RNI No. **KARBIL/2001/47147**

# ಕರ್ನಾಟಕ ರಾಜ್ಯಪತ್ರ

**ಅಧಿಕೃತವಾಗಿ ಪ್ರಕಟಿಸಲಾದುದು**

| ಸಂಪುಟ ೧೪೮<br>Volume 148 | ಬೆಂಗಳೂರು, ಗುರುವಾರ, ಮಾರ್ಚ್ ೭, ೨೦೧೩ (ಫಾಲ್ಗುಣ ೧೬, ಶಕ ವರ್ಷ ೧೯೩೪)<br>Bangalore, Thursday, March 7, 2013 (Phalguna 16, Shaka Varsha 1934) | ಸಂಚಿಕೆ ೧೦<br>Issue 10 |
|---|---|---|

## ಭಾಗ – ೧

## ರಾಜ್ಯ ಸರ್ಕಾರದ ಮುಖ್ಯ ಆದೇಶಗಳು ಹಾಗೂ ಸುತ್ತೋಲೆ ಮುಂತಾದ ಎಲ್ಲಾ ಇಲಾಖೆಗಳಿಗೂ ಸಂಬಂಧಿಸಿದ ಆದೇಶಗಳು

### ಒಳಾಡಳಿತ ಸಚಿವಾಲಯ

**ವಿಷಯ :** ಶ್ರೀ ಅಬ್ದುಲ್ ಖಾದರ್, ಪಿ.ಐ., ಮತ್ತು ಶ್ರೀ ಬೀರಯ್ಯ, ವೈಯ್ಯಾಲಿ ಕಾವಲ್ ಪೊಲೀಸ್ ಠಾಣೆ, ಬೆಂಗಳೂರು, ಇವರುಗಳು ಸರ್ಕಾರಕ್ಕೆ ಸಲ್ಲಿಸಿದ ಪರಿಷ್ಕರಣ ಮೇಲ್ಮನವಿ ಕುರಿತು ಅಂತಿಮ ಆದೇಶ.

**ಓದಲಾಗಿದೆ :**

1. ಶಿಸ್ತು ಪ್ರಾಧಿಕಾರ ಹಾಗೂ ಪೊಲೀಸ್ ಆಯುಕ್ತರು, ಬೆಂಗಳೂರು, ಇವರ ಆದೇಶ ಸಂಖ್ಯೆ: ಡಿಇ(2)76/ಸಿಓಪಿ/ಆರ್–7/2010 ದಿನಾಂಕ: 03–9–2010
2. ಮೇಲ್ಮನವಿ ಪ್ರಾಧಿಕಾರ ಹಾಗೂ ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಆದೇಶ ಸಂಖ್ಯೆ: (i) ಸಿಬಿ(8)74/2010–11 ದಿನಾಂಕ: 07–3–2011 (ii) ಅಪೀಲು(4)38/2010–11 (ಓ.ಬಿ. ಸಂಖ್ಯೆ: 46/2010–11) ದಿನಾಂಕ: 17–3–2011
3. ಅರ್ಜಿದಾರರುಗಳ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 03–9–2011 ಮತ್ತು 05–11–2011
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಸಿಬಿ(8)74/2010–11 ದಿನಾಂಕ: 17–02–2012
5. ಕರ್ನಾಟಕ ಲೋಕಸೇವಾ ಆಯೋಗದ ಪತ್ರ ಸಂಖ್ಯೆ: ಪಿಎಸ್‌ಸಿ 91 ಸಿಎನ್‌ಎಸ್ 2012 ದಿನಾಂಕ: 11–9–2012

**ಪ್ರಸ್ತಾವನೆ:**

ಶ್ರೀ ಅಬ್ದುಲ್ ಖಾದರ್, ಪೊಲೀಸ್ ಇನ್ಸ್‌ಪೆಕ್ಟರ್ ಹಾಗೂ ಶ್ರೀ ಬೀರಯ್ಯ ಹೆಚ್.ಸಿ ಇವರುಗಳು ಬೆಂಗಳೂರಿನ ವೈಯಾಲಿ ಕಾವಲ್ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ, ಬೇಜವಾಬ್ದಾರಿತನ ಹಾಗೂ ದುರ್ನಡತೆ ಪ್ರದರ್ಶಿಸಿದ ಕಾರಣದ ಮೇಲೆ ಇವರುಗಳ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು 1965ರ ನಿಯಮ 7 ರಡಿ ಪ್ರತ್ಯೇಕವಾಗಿ ದೋಷಾರೋಪಣೆಯನ್ನು ಹೊರಡಿಸಲಾಗಿದೆ.

**ದೋಷಾರೋಪಣೆ:–**

**(i) ಶ್ರೀ ಅಬ್ದುಲ್ ಖಾದರ್, ಪಿ.ಐ.:–**

ಶ್ರೀ ಅಬ್ದುಲ್ ಖಾದರ್, ಪಿ.ಐ. ವೈಯಾಲಿ ಕಾವಲ್ ಪೊಲೀಸ್ ಠಾಣೆ, ಬೆಂಗಳೂರು ನಗರದಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ದಿನಾಂಕ: 10–04–10 ರಂದು ಶ್ರೀ ಬೀರಯ್ಯ, ಹೆಚ್.ಸಿ.2653 ರವರನ್ನು ರಾತ್ರಿ ಕರ್ತವ್ಯದ ಪ್ರಭಾರವನ್ನು ವಹಿಸಿಕೊಳ್ಳಲು ತಿಳಿಸಿರುತ್ತೀರಿ, ಸದರಿ ಹೆಚ್.ಸಿ. ರವರು ರಾತ್ರಿ ಕರ್ತವ್ಯವನ್ನು ವಹಿಸಿಕೊಳ್ಳಲು ತಿರಸ್ಕರಿಸಿರುತ್ತಾರೆ. ನಂತರ ಠಾಣಾಧಿಕಾರಿಯಾದ ನೀವು ಸದರಿ ಹೆಚ್.ಸಿ. ರವರು ಕರ್ತವ್ಯವನ್ನು ನಿರಾಕರಿಸಿದ್ದಲ್ಲಿ ನೀವು ಹೆಚ್.ಸಿ. ಶ್ರೀ ಬೀರಯ್ಯ ರವರ ವಿರುದ್ಧ ವರದಿಯನ್ನು ಎ.ಸಿ.ಪಿ./ಡಿಸಿಪಿ ರವರಿಗೆ ಕಳುಹಿಸಬಹುದಿತ್ತು, ವಿನಾಕಾರಣ ಹೆಚ್.ಸಿ. ರವರ ವಿರುದ್ಧ ವಾಗ್ವಾದಕ್ಕಿಳಿದು ಅವರಿಗೆ ಹೊಡೆದು ಅವಾಚ್ಯ ಶಬ್ದಗಳಿಂದ ಬೈದಿರುತ್ತೀರಿ ಈ ರೀತಿ ಒಬ್ಬ ಜವಾಬ್ದಾರಿಯುತ ಠಾಣಾಧಿಕಾರಿಯಾದ ನೀವು ಠಾಣೆಯ ಸಿಬ್ಬಂದಿಗಳೊಂದಿಗೆ ಅಸಭ್ಯತೆಯಿಂದ ವರ್ತಿಸಿ ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ, ಬೇಜವಾಬ್ದಾರಿತನ ಹಾಗೂ ದುರ್ನಡತೆ ಪ್ರದರ್ಶಿಸಿರುತ್ತೀರಿ.

**(ii) ಶ್ರೀ ಬೀರಯ್ಯ, ಹೆಚ್.ಸಿ.:–**

ಶ್ರೀ ಬೀರಯ್ಯ, ಹೆಚ್.ಸಿ. 2653 ಆದ ನೀವು ವೈಯಾಲಿ ಕಾವಲ್ ಪೊಲೀಸ್ ಠಾಣೆ, ಬೆಂಗಳೂರು ನಗರದಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ದಿನಾಂಕ: 10–4–10 ರಂದು ರಾತ್ರಿ ಶ್ರೀ ಚಿಕ್ಕಚೌಡಪ್ಪ, ಎ.ಎಸ್.ಐ. ರವರು ತಮ್ಮ ಹಗಲು ಕರ್ತವ್ಯ ಮುಗಿಸಿ ರಾತ್ರಿ ಕರ್ತವ್ಯಕ್ಕೆ ಸಿಬ್ಬಂದಿಗಳಿಗೆ ರೋಲ್‌ಕಾಲ್ ಮಾಡಿ ಠಾಣೆಯಲ್ಲಿರುವ ರೂಢಿಯಂತೆ ಆ ದಿನದ ರಾತ್ರಿ ಕರ್ತವ್ಯಕ್ಕೆ ಪ್ರಭಾರಕ್ಕೆ ನಿಮ್ಮನ್ನು ನೇಮಿಸಿ ಠಾಣಾ ದಿನಚರಿಯನ್ನು ಪಡೆಯಲು ಹೇಳಿದಾಗ ನೀವು ಠಾಣಾ ಪ್ರಭಾರದ ಕರ್ತವ್ಯವನ್ನು ವಹಿಸಿಕೊಳ್ಳಲು ತಿರಸ್ಕರಿಸಿರುತ್ತೀರಿ ನಂತರ ಠಾಣಾಧಿಕಾರಿಯವರು ದೂರವಾಣಿ ಮೂಲಕ ಠಾಣಾ ಪ್ರಭಾರವನ್ನು ವಹಿಸಿಕೊಳ್ಳುವಂತೆ ಸೂಚಿಸಿದರೂ ಸಹಾ ಪಿ.ಐ. ರವರ ಸೂಚನೆಯನ್ನು ತಿರಸ್ಕರಿಸಿ ನನಗೆ ಬೇರೆ ಕರ್ತವ್ಯವನ್ನು ಕೊಡುವಂತೆ ಕೇಳಿಕೊಂಡಿರುತ್ತೀರಿ. ಈ ರೀತಿ ಠಾಣಾ ಪ್ರಭಾರದ ಜವಾಬ್ದಾರಿ ಹೊಂದಿರುವ ಪಿ.ಐ. ರವರು ನೀಡಿದ ಕಾನೂನು ಬದ್ಧ ಸೂಚನೆಗಳನ್ನು ತಿರಸ್ಕರಿಸಿ ನಿಮ್ಮ ಕರ್ತವ್ಯದಲ್ಲಿ ಅತೀವ ನಿರ್ಲಕ್ಷತೆ, ಬೇಜವಾಬ್ದಾರಿತನ ಹಾಗೂ ದುರ್ನಡತೆಯನ್ನು ಪ್ರದರ್ಶಿಸಿರುತ್ತೀರಿ.

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರುಗಳ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತುಪ್ರಾಧಿಕಾರಿ ಹಾಗೂ ಪೊಲೀಸ್ ಆಯುಕ್ತರು, ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 03–09–2010ರ ಆದೇಶದಲ್ಲಿ ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ಮುಂದಿನ ವಾರ್ಷಿಕ ವೇತನ ಬಡ್ತಿಗಳಿಗೆ ದಕ್ಕೆಯಾಗದಂತೆ 2 ವರ್ಷಕಾಲ ಮುಂದೂಡಲಾದ ದಂಡನೆಯನ್ನು ವಿಧಿಸಿದ್ದಾರೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ನೃಪತುಂಗ ರಸ್ತೆ, ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: ದಿನಾಂಕ: 07–03–2011 ಮತ್ತು 17–03–2011ರ ಆದೇಶಗಳಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಅರ್ಜಿದಾರರಿಗೆ ವಿಧಿಸಿದ ದಂಡನೆಯು ಆರೋಪಕ್ಕೆ ಅನುಗುಣವಾಗಿಲ್ಲವೆಂದು ಪರಿಗಣಿಸಿ, ಶಿಸ್ತು ಪ್ರಾಧಿಕಾರದ ದಂಡನಾದೇಶವನ್ನು ಭಾಗಶಃ ಮಾರ್ಪಡಿಸುವ ಕುರಿತಂತೆ ಓದಲಾದ (5)ರ ಪತ್ರದಲ್ಲಿ ಕರ್ನಾಟಕ ಲೋಕಸೇವಾ ಆಯೋಗದ ಸಹಮತಿಯನ್ನು ಪಡೆದು ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 120 ಪೊಸಿಅ 2011 ಬೆಂಗಳೂರು, ದಿನಾಂಕ: 29–9–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಅಬ್ದುಲ್ ಖಾದರ್, ಪಿ.ಐ., ಮತ್ತು ಶ್ರೀ ಬೀರಯ್ಯ, ಸಿ.ಹೆಚ್.ಸಿ., ವೈಯ್ಯಾಲಿ ಕಾವಲ್ ಪೊಲೀಸ್ ಠಾಣೆ, ಬೆಂಗಳೂರು, ಇವರುಗಳಿಗೆ ಶಿಸ್ತು ಪ್ರಾಧಿಕಾರದ ದಿನಾಂಕ: 03–9–2010ರ ಆದೇಶದಲ್ಲಿ ವಿಧಿಸಿದ ದಂಡನೆಯನ್ನು ಭಾಗಶಃ ಮಾರ್ಪಡಿಸಿ ಇವರುಗಳ ವಾರ್ಷಿಕ ವೇತನ ಬಡ್ತಿಯನ್ನು ಒಂದು ವರ್ಷ ಕಾಲ ಮುಂದಿನ ವಾರ್ಷಿಕ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ ಮುಂದೂಡುವ ದಂಡನೆಯನ್ನು ವಿಧಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

PR 20

**ಒಳಾಡಳಿತ ಸಚಿವಾಲಯ**

**ವಿಷಯ:** ಶ್ರೀ ಜಿ. ಕಾಶೀನಾಥ, ಪಿ.ಎಸ್.ಐ., ಹೊಸಪೇಟೆ ಬಡಾವಣೆ ಪೊಲೀಸ್ ಠಾಣೆ, ಬಳ್ಳಾರಿ ಜಿಲ್ಲೆ, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಬಳ್ಳಾರಿ, ಇವರ ಆದೇಶ ಸಂಖ್ಯೆ: 23/ಪಿಆರ್/2011 (ಜಿ.ಆ. ಸಂಖ್ಯೆ: 214/2011) ದಿನಾಂಕ: 10–6–2011
2. ಮೇಲ್ಮನವಿ ಪ್ರಾಧಿಕಾರ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರ ಆದೇಶ ಸಂಖ್ಯೆ: 32/ಅಪೀಲು/ಸಿಬ್ಬಂದಿ–2/ 2011–12 (ಓ.ಬಿ. 149/11–12) ದಿನಾಂಕ: 28–12–2011
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 20–01–2012
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)65/2011–12 ದಿನಾಂಕ: 31–3–2012

**ಪ್ರಸ್ತಾವನೆ:**

ಶ್ರೀ ಜಿ. ಕಾಶೀನಾಥ, ಪಿ.ಎಸ್.ಐ., ಹೊಸಪೇಟೆ ಬಡಾವಣೆ ಪೊಲೀಸ್ ಠಾಣೆ, ಇವರು (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ನಿರ್ಲಕ್ಷತನ ಮತ್ತು ಬೇಜವಾಬ್ದಾರಿತನ ಪ್ರದರ್ಶಿಸಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು, 1965ರ ನಿಯಮ 7 ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

"ಶ್ರೀ ಜಿ. ಕಾಶೀನಾಥ್, ಪಿ.ಎಸ್.ಐ. ಆದ ನೀವು ಹೊಸಪೇಟೆ ಬಡಾವಣೆ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿರುವಿರಿ. ಶ್ರೀ ಹೇಮಂತ್ ಎಸ್. ಜೈನ್ ತಂದೆ ಸುಭಾಸ್ ಜೈನ್, ಎಂ.ಜಿ. ರಸ್ತೆ, ಹೊಸಪೇಟೆ ರವರು ತಮ್ಮ ತಂದೆ ಸುಭಾಸ್ ಜೈನ್ ರವರನ್ನು ಅಪಹರಣ ಮಾಡಿದ್ದು, ಈ ಬಗ್ಗೆ ಬಡಾವಣೆ ಠಾಣೆಯಲ್ಲಿ ದಿನಾಂಕ: 15–12–2010 ರಂದು ಪ್ರಕರಣ ದಾಖಲಾಗಿರುತ್ತದೆ. ಈ ಪ್ರಕರಣ ವರದಿಯಾಗಿ ನಾಲ್ಕು ತಿಂಗಳು ನಡೆದರೂ ಸಹ ಕೃತ್ಯ ನಡೆದ ಸ್ಥಳದ ಪಂಚನಾಮೆ ಹಾಗೂ ಇತರೆ ಸಾಕ್ಷಿದಾರರುಗಳ ಹೇಳಿಕೆಗಳನ್ನು ಮಾಡದೇ ಅಪಹರಣಕ್ಕೆ ಒಳಗಾದ ಸುಭಾಸ್ ಜೈನ್ ರವರ ಹೇಳಿಕೆಯನ್ನು ಸಹ ಪಡೆದಿರುವುದಿಲ್ಲ & ಬರ್ಕೆ ಪೊಲೀಸ್ ಠಾಣೆಯ ಪಿ.ಎಸ್.ಐ. & ಅವರ ಜೊತೆಗಿದ್ದ 4 ಜನರ ಹೇಳಿಕೆಗಳನ್ನು ಸಹ ಪಡೆದಿರುವುದಿಲ್ಲ. ಈ ಬಗ್ಗೆ ಅಪರಾಧ ಸಭೆಯಲ್ಲಿ ಸೂಚನೆ & ಆದೇಶಗಳನ್ನು ನೀಡಿದರೂ ಮೇಲಾಧಿಕಾರಿಗಳ ಆದೇಶವನ್ನು ಪಾಲಿಸಿರುವುದಿಲ್ಲವೆಂದು ಉಲ್ಲೇಖಿತ ವರದಿಯಿಂದ ತಿಳಿದು ಬಂದಿರುತ್ತದೆ.

ಶಿಸ್ತು ಇಲಾಖೆಯಲ್ಲಿ ನೀವು ಒಬ್ಬ ಉನ್ನತ ಅಧಿಕಾರಿಯಾಗಿದ್ದುಕೊಂಡು, ಅಪರಾಧ ಪ್ರಕರಣಗಳು ದಾಖಲಾತಿ ಆದ ಕೂಡಲೇ ನ್ಯಾಯಸಮ್ಮತ ರೀತಿಯಲ್ಲಿ ತನಿಖೆ ಮಾಡುವುದು & ತನಿಖೆಯ ಬಗ್ಗೆ ಮೇಲಾಧಿಕಾರಿಗಳಿಂದ ಸೂಕ್ತ ಸಲಹೆ & ಸೂಚನೆಗಳನ್ನು ಪಡೆಯುವುದು ನಿಮ್ಮ ಆದ್ಯ ಕರ್ತವ್ಯವಾಗಿರುತ್ತದೆ. ಆದರೆ, ನೀವು ಹಾಗೆ ಮಾಡದೇ, ಸದರಿ ಪ್ರಕರಣದ ತನಿಖೆಯಲ್ಲಿ ಕರ್ತವ್ಯ ನಿರ್ಲಕ್ಷತನ ಮತ್ತು ಬೇಜವಾಬ್ದಾರಿತನ ತೋರಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಬಳ್ಳಾರಿ, ಇವರು ಮೇಲೆ ಕ್ರಮ ಸಂಖ್ಯೆ: (1)ರಲ್ಲಿ ಓದಲಾದ ದಿನಾಂಕ: 10–6–2011ರ ಆದೇಶದಲ್ಲಿ ಅರ್ಜಿದಾರರ ವಾರ್ಷಿಕ ವೇತನ ಬಡ್ತಿಯನ್ನು ಮುಂದಿನ ವಾರ್ಷಿಕ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ ಆರು ತಿಂಗಳ ಕಾಲ ಮುಂದೂಡಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 28–12–2011ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಕರ್ತವ್ಯದಲ್ಲಿ ನಿರ್ಲಕ್ಷತನ ಮತ್ತು ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 5 ಪೊಸಿಅ 2012 ಬೆಂಗಳೂರು, ದಿನಾಂಕ: 05–7–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಜಿ. ಕಾಶೀನಾಥ, ಪಿ.ಎಸ್.ಐ., ಹೊಸಪೇಟೆ ಬಡಾವಣೆ ಪೊಲೀಸ್ ಠಾಣೆ, ಬಳ್ಳಾರಿ ಜಿಲ್ಲೆ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

**P R 24**

## ಒಳಾಡಳಿತ ಸಚಿವಾಲಯ

**ವಿಷಯ:** ಶ್ರೀ ನಾರಾಯಣಸ್ವಾಮಿ, ಮಾಜಿ ಪಿ.ಸಿ.–9558, ಹೈಗ್ರೌಂಡ್ಸ್ ಪೊಲೀಸ್ ಠಾಣೆ, ಬೆಂಗಳೂರು, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಪೊಲೀಸ್ ಆಯುಕ್ತರು, ಬೆಂಗಳೂರು ನಗರ ಇವರ ಆದೇಶ ಸಂಖ್ಯೆ: 05/ಡಿಇ–1/ಆರ್.6/2009 ದಿನಾಂಕ: 13–4–2010
2. ಮೇಲ್ಮನವಿ ಪ್ರಾಧಿಕಾರ ಹಾಗೂ ಡಿ.ಜಿ. ಮತ್ತು ಐ.ಜಿ.ಪಿ. ಬೆಂಗಳೂರು, ಇವರ ಆದೇಶ ಸಂಖ್ಯೆ: ಅಪೀಲು(4)/07/2010–11 (ಓ.ಬಿ. ಸಂಖ್ಯೆ: 23/ 2010–11) ದಿನಾಂಕ: 16–9–10
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 09–01–2012
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)70/2011–12 ದಿನಾಂಕ: 18–4–2012

**ಪ್ರಸ್ತಾವನೆ:**

ಶ್ರೀ ನಾರಾಯಣಸ್ವಾಮಿ, ಇವರು ಬೆಂಗಳೂರಿನ ಹೈಗ್ರೌಂಡ್ ಪೊಲೀಸ್ ಠಾಣೆಯಲ್ಲಿ ಪೊಲೀಸ್ ಕಾನ್ಸ್‌ಟೇಬಲ್ ಆಗಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ದರೋಡೆ ನಡೆಸಿ ಕರ್ತವ್ಯದಲ್ಲಿ ಅತೀವ ನಿರ್ಲಕ್ಷತೆ, ಅಧಿಕಾರ ದುರುಪಯೋಗಪಡಿಸಿಕೊಂಡು ಇಲಾಖೆಯ ಘನತೆಗೆ ದಕ್ಕೆ ತಂದ ಕಾರಣದ ಮೇಲೆ ಇನ್ನಿಬ್ಬರು ಪೊಲೀಸ್ ಕಾನ್ಸ್‌ಟೇಬಲ್ ರವರೊಂದಿಗೆ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು, 1965ರ ನಿಯಮ 6 ಮತ್ತು 8 ರೊಂದಿಗೆ ಜಂಟಿ ಇಲಾಖಾ ವಿಚಾರಣೆಗೆ ಆದೇಶಿಸಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

> "ಶ್ರೀ ನಾರಾಯಣಸ್ವಾಮಿ ಪಿ.ಸಿ. 9558 ಮತ್ತು ಶ್ರೀ ಪ್ರಸನ್ನ ಪಿ.ಸಿ. 9563, ಆದ ನೀವು ಹೈಗ್ರೌಂಡ್ ಪೊಲೀಸ್ ಠಾಣೆ ಹಾಗೂ ಶ್ರೀ ಅಶ್ವಥ್ ರೆಡ್ಡಿ ಪಿ.ಸಿ. 9618, ಮಹಿಳೆ ಮತ್ತು ಮಾದಕ ದ್ರವ್ಯ ದಳ, ಸಿ.ಸಿ.ಬಿ. ಬೆಂಗಳೂರು ನಗರ ಇಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದೀರಿ. ನೀವುಗಳು ದಿ: 19–02–2008 ರಂದು ರಾತ್ರಿ ಸುಮಾರು 9–30 ಗಂಟೆ ಸಮಯದಲ್ಲಿ ಸಾರ್ವಜನಿಕರಾದ ಶ್ರೀನಿವಾಸ್, ಸುಧಾಕರ ರೆಡ್ಡಿ ಹಾಗೂ ವೆಂಕಟನಾರಾಯಣ ಎಂಬುವವರೊಂದಿಗೆ ಸೇರಿಕೊಂಡು ಸಂಚು ನಡೆಸಿ, ಒಂದು ಟಾಟಾ ಸುಮೋದಲ್ಲಿ ಪಿರ್ಯಾದುದಾರರಾದ ಶ್ರೀ ಸಂಜೀವ್ ಎ ಕುರುಪ್, ನಂ.ಸಿ.–66, ಕೆ.ಪಿ.ಡಬ್ಲ್ಯೂಡಿ ಕ್ವಾಟ್ರಸ್, ಜೀವನಭೀಮನಗರ, ಬೆಂಗಳೂರು 75 ರವರ ಮನೆಗೆ ಅಕ್ರಮ ಪ್ರವೇಶ ಮಾಡಿ, ಶಿವಮೊಗ್ಗ ಪೊಲೀಸರೆಂದು ಸುಳ್ಳು ಹೇಳಿ ಶ್ರೀ ಸಂಜೀವ್ ಎ ಕುರುಪ್ ರವರ ಕೈಗೆ ಬೇಡಿ ತೊಡಿಸಿ ಅವರ ಮನೆಯಲ್ಲಿದ್ದ ಬೆಲೆ ಬಾಳುವ ಒಂದು ಹಳೇ ದೇವರ ಫೋಟೋವನ್ನು ಬಲವಂತವಾಗಿ ವಶಕ್ಕೆ ಪಡೆದು ನಂತರ ಶ್ರೀ ಸಂಜೀವ್ ಎ ಕುರುಪ್ ಹಾಗೂ ಅವರ ಪತ್ನಿಯನ್ನು ಸದರಿ ಟಾಟಾ ಸುಮೋ ವಾಹನದಲ್ಲಿ ಕುಳ್ಳಿರಿಸಿಕೊಂಡು ಹೋಗಿ ಏರ್‌ಪೋರ್ಟ್ ರಸ್ತೆಯಲ್ಲಿ ಟಾಟಾ ಸುಮೋದಿಂದ ಅವರಿಬ್ಬರನ್ನು ಕೆಳಗೆ ಇಳಿಸಿ ನೀವು ಪರಾರಿಯಾಗಿರುತ್ತೀರಿ. ನೀವು ಪೊಲೀಸ್ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಸಾರ್ವಜನಿಕರ ರಕ್ಷಣೆ ಅಪರಾಧ ತಡೆಯುವುದು ಅಪರಾಧಿಗಳನ್ನು ಪತ್ತೆಹಚ್ಚುವ ಕಾರ್ಯ ನಿರ್ವಹಿಸ–ಬೇಕಾಗಿದ್ದರೂ ಸಹ ನೀವುಗಳೇ ದರೋಡೆ ನಡೆಸಿ, ನಿಮ್ಮ ಕರ್ತವ್ಯದಲ್ಲಿ ಅತೀವ ನಿರ್ಲಕ್ಷ್ಯತೆ, ಅಧಿಕಾರ ದುರುಪಯೋಗ ಹಾಗೂ ಗಂಭೀರ ಸ್ವರೂಪದ ಕರ್ತವ್ಯಲೋಪವೆಸಗಿ ಪೊಲೀಸ್ ಇಲಾಖೆಯ ಘನತೆಗೆ ಧಕ್ಕೆ ತಂದಿರುತ್ತೀರಿ. ಈ ಬಗ್ಗೆ ಶ್ರೀ ಸಂಜೀವ್ ಎ ಕುರುಪ್ ರವರು ನೀಡಿದ ದೂರಿನ ಮೇರೆಗೆ ನಿಮ್ಮ ವಿರುದ್ದ ಜೆ.ಬಿ. ನಗರ ಪೊಲೀಸ್ ಠಾಣೆಯಲ್ಲಿ ಮೊ.ಸಂ. 78/08, ಕಲಂ 419–420–120(ಬಿ) 395 ಐಪಿಸಿ ಪ್ರಕಾರ ಪ್ರಕರಣ ದಾಖಲಾಗಿರುತ್ತದೆ."

ಮೇಲ್ಕಂಡ ಆರೋಪದ ಮೇಲೆ ಜಂಟಿ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ ಸಾಬೀತಾಗಿದೆ ಎಂದು ಸಲ್ಲಿಸಿದ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಪೊಲೀಸ್ ಆಯುಕ್ತರು, ಬೆಂಗಳೂರು ನಗರ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 13–4–2010ರ ಆದೇಶದಲ್ಲಿ ಅರ್ಜಿದಾರರನ್ನು ಸೇವೆಯಿಂದ ವಜಾಗೊಳಿಸಲಾಗಿದೆ ದಿನಾಂಕ: 28–01–2009 ರಿಂದ ಸದರಿ ಆದೇಶ ಹೊರಡಿಸಿದ ದಿನಾಂಕದವರೆಗಿನ ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೆ ಪರಿಗಣಿಸಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಡಿ.ಜಿ. ಮತ್ತು ಐ.ಜಿ.ಪಿ. ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 16–9–2010ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ಇಲಾಖಾ ವಿಚಾರಣೆ ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ, ಕರ್ತವ್ಯದಲ್ಲಿದ್ದಾಗ ದರೋಡೆ ನಡೆಸಿ ಕರ್ತವ್ಯದಲ್ಲಿ ಅತೀವ ನಿರ್ಲಕ್ಷತೆ, ಅಧಿಕಾರ ದುರುಪಯೋಗಪಡಿಸಿಕೊಂಡಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 15 ಪೊಸಿಅ 2012 ಬೆಂಗಳೂರು, ದಿನಾಂಕ: 05–7–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ನಾರಾಯಣಸ್ವಾಮಿ, ಮಾಜಿ ಪಿ.ಸಿ.–9558, ಹೈಗ್ರೌಂಡ್ಸ್ ಪೊಲೀಸ್ ಠಾಣೆ, ಬೆಂಗಳೂರು, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

P R 25

## ಒಳಾಡಳಿತ ಸಚಿವಾಲಯ

**ವಿಷಯ:** ಶ್ರೀ ಎಸ್.ಬಿ. ಛಬ್ಬಿ, ಪಿ.ಐ., ಗಂಗಮ್ಮನಗುಡಿ ಪೊಲೀಸ್ ಠಾಣೆ, ಬೆಂಗಳೂರು, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಉಪ ಪೊಲೀಸ್ ಅಯುಕ್ತರು, ಪೂರ್ವ ವಿಭಾಗ, ಬೆಂಗಳೂರು, ಇವರ ಆದೇಶ ಸಂಖ್ಯೆ: 96/ಡಿ.ಇ/ಆರ್–7/ಪೂ/2007 ದಿನಾಂಕ: 31–12–2007
2. ಮೇಲ್ಮನವಿ ಪ್ರಾಧಿಕಾರ ಹಾಗೂ ಅಡಿಷನಲ್ ಪೊಲೀಸ್ ಆಯುಕ್ತರು, ಆಡಳಿತ, ಬೆಂಗಳೂರು ನಗರ, ಇವರ ಆದೇಶ ಸಂಖ್ಯೆ: 22/ಅಪೀಲು/ 2008 ದಿನಾಂಕ: 26–8–2009
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 22–10–2009
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಸಿಬಿ(8)/106/2009–10 ದಿನಾಂಕ: 01–8–2011

**ಪ್ರಸ್ತಾವನೆ:**

ಶ್ರೀ ಎಸ್.ಬಿ. ಛಬ್ಬಿ, ಪಿ.ಐ., ಇವರು ಬೆಂಗಳೂರಿನ ಗಂಗಮ್ಮನ ಗುಡಿ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ, ಅಶಿಸ್ತು ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿದ ಕಾರಣದ ಮೇಲೆ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು, 1965ರ ನಿಯಮ 7 ರಡಿ ಈ ಕೆಳಕಂಡ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

> "ಈ ದಿನ ಠಾಣೆಗೆ ಭೇಟಿ ನೀಡಿ ತನಿಖೆಯಲ್ಲಿರುವ ಪ್ರಕರಣಗಳಲ್ಲಿ ಯು.ಡಿ.ಅರ್. ನಂ. 25/07 ಕಲಂ 174 ಸಿ.ಆರ್.ಪಿ.ಸಿ. ಕೇಸಿನ ಕಡತವನ್ನು ಪರಿಶೀಲಿಸಲಾಗಿ ದಿನಾಂಕ: 18–7–07 ರಂದು ಫಿರ್ಯಾದಿ ಶ್ರೀ ಬಬ್ಲೂ ಕುಮಾರ್ ಮೈಸೋರ್ ಬಿನ್ ರಮೇಶ್ ಮೈಸೋರೆ ಎಂಬುವವರು ನೀಡಿರುವ ಹೇಳಿಕೆ ದೂರಿನಲ್ಲಿ ಪಿರ್ಯಾದಿಯ ತಮ್ಮ ಜಿತೇಂದ್ರ ಕಟ್ಟಡ ಕೆಲಸ ಮಾಡುತ್ತಾ ಸೆಂಟ್ರಿಂಗ್ ತೆಗೆಯುವಾಗ್ಗೆ 3ನೇ ಮಹಡಿಯಿಂದ ಕೆಳಗೆ ಬಿದ್ದು ಮೃತಪಟ್ಟಿದ್ದಾಗಿ ತಿಳಿಸಿರುತ್ತಾರೆ. ಪಿರ್ಯಾದಿಯ ಹೇಳಿಕೆಯಿಂದ ಈ ಘಟನೆಯಲ್ಲಿ ಕಟ್ಟಡ ನಿರ್ಮಾಣದವರ ನಿರ್ಲಕ್ಷತೆಯಿಂದ ಫಿರ್ಯಾದಿಯ ತಮ್ಮ ಮೃತಪಟ್ಟಿರುವುದು ಕಂಡುಬರುತ್ತದೆ. "ಫಿರ್ಯಾದಿಯ ಹೇಳಿಕೆಯಿಂದ ಈ ಘಟನೆಯು ಕಲಂ 304(ಎ) ಐಪಿಸಿ ಅಡಿಯಲ್ಲಿ ಅಪರಾಧವಾಗಿರುವುದು ಸ್ಪಷ್ಟವಾಗಿದ್ದರು" ಕೂಡಾ ಪಿ.ಎಸ್.ಐ. ರವರು ಕಲಂ 304(ಎ) ಐಪಿಸಿ ಅಡಿಯಲ್ಲಿ ಪ್ರಕರಣ ದಾಖಲು ಮಾಡಿ ತನಿಖೆಯನ್ನು ನಡೆಸದೆ ಯು.ಡಿ.ಆರ್. ಪ್ರಕರಣ ದಾಖಲು ಮಾಡಿರುತ್ತಾರೆ.
>
> ನೀವು ಠಾಣಾಧಿಕಾರಿಯಾಗಿ ನಿಮ್ಮ ಅಧೀನ ಅಧಿಕಾರಿಯಾದ ಪಿ.ಎಸ್.ಐ. ರವರ ಕರ್ತವ್ಯಗಳನ್ನು ಪರಿಶೀಲಿಸಿ ಪಿ.ಎಸ್.ಐ. ರವರು ಆರೋಪಿಗಳೊಂದಿಗೆ ಶಾಮೀಲಾಗಿ ಸಂಜ್ಞೇಯ ಅಪರಾಧವನ್ನು ಮುಚ್ಚಿಹಾಕಿರುವುದನ್ನು ಪರಿಶೀಲಿಸಿ ಅವರ ತನಿಖೆಯಲ್ಲಿನ ನ್ಯೂನತೆಗಳನ್ನು ಸರಿಪಡಿಸುವಲ್ಲಿ ವಿಫಲರಾಗಿ ನಿಮ್ಮ ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ, ಬೇಜವಾಬ್ದಾರಿಯನ್ನು ಪ್ರದರ್ಶಿಸಿರುತ್ತೀರಾ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಉಪ ಪೊಲೀಸ್ ಅಯುಕ್ತರು, ಪೂರ್ವ ವಿಭಾಗ, ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ: (1)ರಲ್ಲಿ ಓದಲಾದ ದಿನಾಂಕ: 31–12–2007ರ ಆದೇಶದಲ್ಲಿ ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು 6 ತಿಂಗಳ ಕಾಲ ನಂತರದ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ ಮುಂದೂಡಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಅಡಿಷನಲ್ ಪೊಲೀಸ್ ಆಯುಕ್ತರು, ಆಡಳಿತ, ಬೆಂಗಳೂರು ನಗರ, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 26–8–2009ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ, ಅಶಿಸ್ತು ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 190 ಪೊಸಿಅ 2009 ಬೆಂಗಳೂರು, ದಿನಾಂಕ: 05–7–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಎಸ್.ಬಿ. ಛಬ್ಬಿ, ಪಿ.ಐ., ಗಂಗಮ್ಮನಗುಡಿ ಪೊಲೀಸ್ ಠಾಣೆ, ಬೆಂಗಳೂರು, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

PR 26

## ಒಳಾಡಳಿತ ಸಚಿವಾಲಯ

**ವಿಷಯ:** ಶ್ರೀ ಜಿ. ಯತಿರಾಜ್, ಎ.ಎಸ್.ಐ., ನ್ಯೂಟೌನ್ ಪೊಲೀಸ್ ಠಾಣೆ, ಭದ್ರಾವತಿ, ಶಿವಮೊಗ್ಗ ಜಿಲ್ಲೆ, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಶಿವಮೊಗ್ಗ, ಇವರ ಆದೇಶ ಸಂಖ್ಯೆ: ಸಿಬ್ಬಂದಿ(7)/ಶಿಕ್ವೆ/100/2010 (ಓ.ಬಿ. 161/2011) ದಿನಾಂಕ: 22–3–2011
2. ಮೇಲ್ಮನವಿ ಪ್ರಾಧಿಕಾರ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರ ಆದೇಶ ಸಂಖ್ಯೆ: 05/ಅಪೀಲು/ಸಿಬ್ಬಂದಿ–2/ 2011–12 (ಓ.ಬಿ. 24/2011–12) ದಿನಾಂಕ: 25–5–2011
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 16–8–2011
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)37/2011–12 ದಿನಾಂಕ: 25–11–2011

**ಪ್ರಸ್ತಾವನೆ:**

ಶ್ರೀ ಜಿ. ಯತಿರಾಜ್, ಎ.ಎಸ್.ಐ., ಇವರು ಶಿವಮೊಗ್ಗ ಮಹಿಳಾ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ತೀವ್ರ ಕರ್ತವ್ಯಲೋಪ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು, 1965ರ ನಿಯಮ 7 ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

> "ಶ್ರೀ ಯತಿರಾಜ್ ಎ.ಎಸ್.ಐ. ಮತ್ತು ಮಹಿಳಾ ಪಿ.ಸಿ.–746, ಶ್ರೀಮತಿ ಸರೋಜಮ್ಮ ಆದ ನೀವುಗಳು ಶಿವಮೊಗ್ಗ ಮಹಿಳಾ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಮಹಿಳಾ ಪೊಲೀಸ್ ಠಾಣೆ ಗುನ್ನೆ ಸಂಖ್ಯೆ: 56/2010 ಕಲಂ: 489(ಎ), 420, 506, 504, 323, ಸಹಿತ 34 ಐ.ಪಿ.ಸಿ. ಪ್ರಕರಣದ ಆರೋಪಿಗಳನ್ನು ಬಂಧಿಸಲು ಟಾಟಾ ಸುಮೋ ವಾಹನದಲ್ಲಿ ಹುಬ್ಬಳ್ಳಿಗೆ ಹೋದ ಸಂದರ್ಭದಲ್ಲಿ ಆರೋಪಿಗಳನ್ನು ಹಿಡಿದು ತಂದು ಠಾಣಾ ಪಿ.ಎಸ್.ಐ. ರವರ ಮುಂದೆ ಹಾಜರುಪಡಿಸದೆ ಅವರನ್ನು ಬಿಟ್ಟು ಕಳಿಸುವ ಮೂಲಕ ತೀವ್ರ ಕರ್ತವ್ಯಲೋಪ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿದ ಆರೋಪಣೆಗಳ ಬಗ್ಗೆ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಶಿವಮೊಗ್ಗ, ಇವರು ಮೇಲೆ ಕ್ರಮ ಸಂಖ್ಯೆ: (1)ರಲ್ಲಿ ಓದಲಾದ ದಿನಾಂಕ: 22–3–2011ರ ಆದೇಶದಲ್ಲಿ ಅರ್ಜಿದಾರರ ವಾರ್ಷಿಕ ವೇತನ ಬಡ್ತಿಯನ್ನು ತದನಂತರದ ವಾರ್ಷಿಕ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ 6 ತಿಂಗಳ ಕಾಲ ಮುಂದೂಡಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 25–5–2011ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ತೀವ್ರ ಕರ್ತವ್ಯಲೋಪ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 90 ಪೊಸಿಅ 2011 ಬೆಂಗಳೂರು, ದಿನಾಂಕ: 05–7–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಯತಿರಾಜ್, ಎ.ಎಸ್.ಐ., ನ್ಯೂಟೌನ್ ಪೊಲೀಸ್ ಠಾಣೆ, ಭದ್ರಾವತಿ, ಶಿವಮೊಗ್ಗ ಜಿಲ್ಲೆ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

P R 27

## ಒಳಾಡಳಿತ ಸಚಿವಾಲಯ

**ವಿಷಯ:** ಶ್ರೀ ಜಿ. ಕಾಶೀನಾಥ, ಪಿ.ಎಸ್.ಐ., ಹೊಸಪೇಟೆ ಬಡಾವಣೆ ಪೊಲೀಸ್ ಠಾಣೆ, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಬಳ್ಳಾರಿ, ಇವರ ಆದೇಶ ಸಂಖ್ಯೆ: 18/ಪಿಆರ್/2011 (ಜಿ.ಆ. ಸಂಖ್ಯೆ: 200/2011) ದಿನಾಂಕ: 03-6-2011
2. ಮೇಲ್ಮನವಿ ಪ್ರಾಧಿಕಾರ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರ ಆದೇಶ ಸಂಖ್ಯೆ: 38/ಅಪೀಲು/ಸಿಬ್ಬಂದಿ-2/ 2011-12 (ಓ.ಬಿ. ಸಂಖ್ಯೆ: 153/2011-12) ದಿನಾಂಕ: 28-12-2011
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 20-01-2012
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)66/2011-12 ದಿನಾಂಕ: 30-3-2012

**ಪ್ರಸ್ತಾವನೆ:**

ಶ್ರೀ ಜಿ. ಕಾಶೀನಾಥ, ಪಿ.ಎಸ್.ಐ., ಹೊಸಪೇಟೆ ಬಡಾವಣೆ ಪೊಲೀಸ್ ಠಾಣೆ, ಇವರು (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ನಿರ್ಲಕ್ಷತನ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು, 1965ರ ನಿಯಮ 7 ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:-**

"ರಹದಾರಿ ಅರ್ಜಿಯನ್ನು ನಿಗದಿತ ಅವಧಿಯೊಳಗೆ ಸಲ್ಲಿಸದೇ ಕರ್ತವ್ಯದಲ್ಲಿ ನಿರ್ಲಕ್ಷತನ ಮತ್ತು ಬೇಜವಾಬ್ದಾರಿತನ ತೋರಿರುವ ಬಗ್ಗೆ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಬಳ್ಳಾರಿ, ಇವರು ಮೇಲೆ ಕ್ರಮ ಸಂಖ್ಯೆ: (1)ರಲ್ಲಿ ಓದಲಾದ ದಿನಾಂಕ: 03-6-2011ರ ಆದೇಶದಲ್ಲಿ ಅರ್ಜಿದಾರರ ವಾರ್ಷಿಕ ವೇತನ ಬಡ್ತಿಯನ್ನು ಮುಂದಿನ ವಾರ್ಷಿಕ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ ಆರು ತಿಂಗಳ ಕಾಲ ಮುಂದೂಡಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 28-12-2011ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಕರ್ತವ್ಯದಲ್ಲಿ ನಿರ್ಲಕ್ಷತನ ಮತ್ತು ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 6 ಪೊಸಿಅ 2012 ಬೆಂಗಳೂರು, ದಿನಾಂಕ: 05-7-2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಜಿ. ಕಾಶೀನಾಥ, ಪಿ.ಎಸ್.ಐ., ಹೊಸಪೇಟೆ ಬಡಾವಣೆ ಪೊಲೀಸ್ ಠಾಣೆ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

P R 28

## ಒಳಾಡಳಿತ ಸಚಿವಾಲಯ

**ವಿಷಯ:** ಶ್ರೀ ಬಿ.ಎಸ್. ಲೋಕಾಪುರ, ಪಿ.ಐ., ಬೆಸ್ಕಾಂ ಯಾದಗಿರಿ ಜಿಲ್ಲೆ, ಯಾದಗಿರಿ, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಬೆಳಗಾಂ, ಇವರ ಆದೇಶ ಸಂಖ್ಯೆ: ಸಿಬ್ಬಂದಿ–2ಎ/ಪಿಆರ್/06/2008 (ಆ.ಪು. ಸಂಖ್ಯೆ: 585/2008) ದಿನಾಂಕ: 25–6–2008
2. ಮೇಲ್ಮನವಿ ಪ್ರಾಧಿಕಾರ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಉತ್ತರ ವಲಯ, ಬೆಳಗಾಂ, ಇವರ ಹಿಂಬರಹ ಸಂಖ್ಯೆ: ಅಪೀಲು/72/ಉವ/2012 ದಿನಾಂಕ: 26–3–2012
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 05–05–2012
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಸಿಬಿ(8)17/2012–13 ದಿನಾಂಕ: 18–7–2012

**ಪ್ರಸ್ತಾವನೆ:**

ಶ್ರೀ ಬಿ.ಎಸ್. ಲೋಕಾಪುರ, ಇವರು ಬೆಳಗಾವಿ ಜಿಲ್ಲೆಯ ರಾಯಭಾಗ ಪೊಲೀಸ್ ಠಾಣೆಯಲ್ಲಿ ಪಿ.ಎಸ್.ಐ. ಆಗಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು 1965ರ ನಿಯಮ 7ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

> "ಆಪಾದಿತ ಪೊಲೀಸ್ ಅಧಿಕಾರಿಯಾದ ನೀವು ರಾಯಭಾಗ ಪೊಲೀಸ್ ಠಾಣೆಯ ಠಾಣಾ ಹದ್ದಿಯಲ್ಲಿ ಮಟಕಾ, ಜೂಜಾಟ ನಿರ್ಮೂಲನೆ ಮಾಡಲು ಮತ್ತು ಕಟ್ಟುನಿಟ್ಟಿನ ಕ್ರಮ ಕೈಕೊಳ್ಳಲು ನಿಮಗೆ ಸೂಚಿಸಿದ್ದರೂ ಸಹ ನಿಮ್ಮ ಠಾಣಾ ವ್ಯಾಪ್ತಿಯಲ್ಲಿ ಅಂತಹ ಮಟಕಾ ಜೂಜಾಟಗಳನ್ನು ನಡೆಯದಂತೆ ಕಟ್ಟುನಿಟ್ಟಿನ ಕ್ರಮವನ್ನು ಕೈಕೊಳ್ಳದೇ ಮತ್ತು ಈ ಬಗ್ಗೆ ನಿಮ್ಮ ಮೇಲಾಧಿಕಾರಿಗಳು ನಿಮಗೆ ನೀಡಿದ ಸೂಕ್ತ ಸಲಹೆ ಸೂಚನೆಗಳನ್ನು ಪಾಲಿಸದೇ ಇರುವುದರಿಂದ ರಾಯಭಾಗ ಠಾಣೆ ಗು.ನಂ. 275/07 ಕಲಂ 78(3) ಕೆ.ಪಿ. ಆಕ್ಟ್ ಅಡಿ ಪ್ರಕರಣ ದಾಖಲಾಗಲು ಕಾರಣೀಭೂತರಾಗಿ ಠಾಣಾ ವ್ಯಾಪ್ತಿಯಲ್ಲಿ ಮಟಕಾ ಜೂಜಾಟವನ್ನು ನಿಯಂತ್ರಿಸುವಲ್ಲಿ ವಿಫಲರಾಗಿ ನಿಮ್ಮ ಕರ್ತವ್ಯದಲ್ಲಿ ಘೋರ ನಿಷ್ಕಾಳಜಿತನ ಹಾಗೂ ಬೇಜವಾಬ್ದಾರಿತನವನ್ನು ಪ್ರದರ್ಶಿಸಿರುವಿರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಬೆಳಗಾಂ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 25–6–2008ರ ಆದೇಶದಲ್ಲಿ ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ಮುಂದಿನ ವಾರ್ಷಿಕ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ 6 ತಿಂಗಳ ಕಾಲ ಮುಂದೂಡಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಉತ್ತರ ವಲಯ, ಬೆಳಗಾಂ, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 26–3–2012ರ ಹಿಂಬರಹದಲ್ಲಿ ಅವಧಿ ಮೀರಿದ ಮೇಲ್ಮನವಿಯೆಂದು ಪರಿಗಣಿಸಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಕರ್ತವ್ಯದಲ್ಲಿ ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

### ಸರ್ಕಾರದ ಆದೇಶ ಸಂಖ್ಯೆ: ಒಇ 48 ಪೊಸಿಅ 2012 ಬೆಂಗಳೂರು, ದಿನಾಂಕ: 16–10–2012

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಬಿ.ಎಸ್. ಲೋಕಾಪುರ, ಪಿ.ಐ., ಯಾದಗಿರಿ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

P R 30

## ಒಳಾಡಳಿತ ಸಚಿವಾಲಯ

**ವಿಷಯ:** ಶ್ರೀ ಹೆಚ್.ಎಸ್. ರಾಮಲಿಂಗೇಗೌಡ, ಪಿ.ಐ., ಸಿಟಿ ಮಾರ್ಕೆಟ್ ಪೊಲೀಸ್ ಠಾಣೆ, ಬೆಂಗಳೂರು ನಗರ, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಪೊಲೀಸ್ ಆಯುಕ್ತರು, ಬೆಂಗಳೂರು ನಗರ, ಇವರ ಆದೇಶ ಸಂಖ್ಯೆ: ಡಿಇ(2)/106/ಸಿಓಪಿ/ಆರ್-7/2010 ದಿನಾಂಕ: 26-11-2010
2. ಮೇಲ್ಮನವಿ ಪ್ರಾಧಿಕಾರ ಹಾಗೂ ಡಿ.ಜಿ. ಮತ್ತು ಐ.ಜಿ.ಪಿ. ಬೆಂಗಳೂರು, ಇವರ ಆದೇಶ ಸಂಖ್ಯೆ: ಸಿಬಿ(8)109/2010-11 ದಿನಾಂಕ: 15-5-2011
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 10-10-2011
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಸಿಬಿ(8)109/2010-11 ದಿನಾಂಕ: 23-5-2012

**ಪ್ರಸ್ತಾವನೆ:**

ಶ್ರೀ ಹೆಚ್.ಎಸ್. ರಾಮಲಿಂಗೇಗೌಡ, ಪಿ.ಐ., ಇವರು ಈ ಹಿಂದೆ ಕೊಡಗು ಜಿಲ್ಲೆಯ ಸೋಮವಾರುಪೇಟೆ ಪೊಲೀಸ್ ಠಾಣೆಯಲ್ಲಿ ಪಿ.ಎಸ್.ಐ. ಆಗಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ, ಬೇಜವಾಬ್ದಾರಿತನ ಹಾಗೂ ಕರ್ತವ್ಯಲೋಪವೆಸಗಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು, 1965ರ ನಿಯಮ 7 ರಡಿ ಈ ಕೆಳಕಂಡ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:-**

"ಶ್ರೀ ಹೆಚ್.ಎಸ್. ರಾಮಲಿಂಗೇಗೌಡ, ಪಿ.ಐ., ಬಸವನಗುಡಿ ಸಂಚಾರ ಪೊಲೀಸ್ ಠಾಣೆ, ಬೆಂಗಳೂರು ನಗರ ಈ ಹಿಂದೆ ಪಿ.ಎಸ್.ಐ. ಸೋಮವಾರಪೇಟೆ ಪೊಲೀಸ್ ಠಾಣೆ, ಕೊಡಗು ಜಿಲ್ಲೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ ನಾಡಪ್ಪ ಎಂಬುವವರು ಶ್ರೀ ಕೆ.ಬಿ. ಮೋಹನ್ @ ಮೋಹನ್ ಕುಮಾರ್ ಬಿನ್ ಬಸಪ್ಪ ಎಂಬುವರು ದಾರಿಯ ವಿಷಯದಲ್ಲಿ ಕೋವಿಯಿಂದ ಹೊಡೆದ ಕಾರಣದಿಂದ ಬಲಭುಜಕ್ಕೆ ಬಲಹೊಟ್ಟೆಗೆ, ಗದ್ದಕ್ಕೆ ಕೋವಿಯ ಚಿಲ್ಲುಗಳು ತಾಗಿ ಗಾಯವಾಗಿರುತ್ತದೆಂದು ನೀಡಿದ ದೂರಿನ ಮೇರೆಗೆ ತನಿಖಾಧಿಕಾರಿಯಾದ ನೀವು ಸೋಮವಾರಪೇಟೆ ಪೊಲೀಸ್ ಠಾಣೆ ಮೊ.ಸಂ. 250/99ರಲ್ಲಿ ಪ್ರಕರಣ ದಾಖಲಿಸಿ ತನಿಖೆ ಪೂರೈಸಿ ಆಪಾದನಾ ಪತ್ರವನ್ನು ನ್ಯಾಯಾಲಯಕ್ಕೆ ಸಲ್ಲಿಸಿರುತ್ತೀರಿ. ಈ ಪ್ರಕರಣದಲ್ಲಿ ಆರೋಪಿತನ ವಶದಿಂದ ಅಮಾನತ್ತುಪಡಿಸಿಕೊಂಡಿದ್ದ ಕೋವಿ ಮತ್ತು ಆತನ ಕೈಯಿಂದ ಗುಂಡು ಹಾರಿಸಿದ ಕಾಟನ್ ಸ್ವಾಬ್, ಘಟನಾ ಸ್ಥಳದಲ್ಲಿನ ಬಿಲೆಟ್‌ಗಳನ್ನು ಅಮಾನತ್ತುಪಡಿಸಿ ತಜ್ಞರಿಗೆ ಪರೀಕ್ಷೆಗಾಗಿ ಕಳುಹಿಸಿದ್ದು, ತಜ್ಞರು ಪರೀಕ್ಷೆಯ ನಂತರ ವರದಿಯೊಂದಿಗೆ ಸದರಿ ಮುದ್ದೆ ಮಾಲುಗಳನ್ನು ಹಿಂದಿರುಗಿಸಿರುತ್ತಾರೆ. ನೀವು ಪರೀಕ್ಷೆಗೆ ಕಳುಹಿಸಿದ್ದ ಬಗ್ಗೆ ವರದಿಯೊಂದಿಗೆ ಅವುಗಳನ್ನು ನವೀಕರಿಸಿದ ಬಗ್ಗೆ ಸಾಕ್ಷ್ಯದಲ್ಲಿ ಏನನ್ನು ನುಡಿದಿರುವುದಿಲ್ಲ. ಅಲ್ಲದೇ ವೈದ್ಯಾಧಿಕಾರಿಗಳು ಜನರಲ್ ಆಸ್ಪತ್ರೆ ಸೋಮವಾರಪೇಟೆ ರವರು ಪ್ರಥಮವಾಗಿ ಗಾಯಾಳುವನ್ನು ಪರೀಕ್ಷಿಸಿ ನಂತರ ಹೆಚ್ಚಿನ ಚಿಕಿತ್ಸೆಗಾಗಿ ಮಂಗಳೂರಿಗೆ ಕಳುಹಿಸಿರುತ್ತಾರೆ. ಆದರೆ ನೀವು ವೈದ್ಯಾಧಿಕಾರಿಗಳಿಂದ ಗಾಯದ ಪ್ರಮಾಣ ಪತ್ರ ಪಡೆದಿರುವುದಿಲ್ಲ. ವೈದ್ಯಾಧಿಕಾರಿಗಳು, ಮಂಗಳೂರು ರವರು ತಮ್ಮ ಸಾಕ್ಷಿಯಲ್ಲಿ ಗಾಯಾಳುವಿನ ಬಲ ಭುಜ ಹಾಗೂ ತಲೆ ಬುರುಡೆ ಎಕ್ಸ್‌ರೇ ತೆಗೆದಿರುವುದಾಗಿ ಇವುಗಳಲ್ಲಿ ಬಿಲೆಟ್ ಇದ್ದುದ್ದು ಕಂಡುಬಂದಿರುತ್ತದೆ ಎಂದು ಸಾಕ್ಷಿಯಲ್ಲಿ ನುಡಿದಿರುತ್ತಾರೆ. ಆದರೆ ನೀವು ಎಕ್ಸ್‌ರೇ ವರದಿಯನ್ನು ವೈದ್ಯರಿಂದ ಪಡೆದು ನ್ಯಾಯಾಲಯದ ಮುಂದೆ ಹಾಜರುಪಡಿಸಿರುವುದಿಲ್ಲ. ಪಾಟಿ ಸವಾಲಿನಲ್ಲಿ ಪೊಲೀಸರು ಎಕ್ಸ್‌ರೇ ವರದಿಗಾಗಿ ತನ್ನನ್ನು ವಿನಂತಿಸಿರುವುದಿಲ್ಲವೆಂದು ನುಡಿದಿರುತ್ತಾರೆ ಹಾಗೂ ಗಾಯಗಳಿಂದ ತೆಗೆದ ಬಿಲೆಟ್‌ಗಳನ್ನು ನೀವು ಸಂಗ್ರಹಿಸಿರುವುದಿಲ್ಲ. ಈ ರೀತಿ ಒಬ್ಬ ಜವಾಬ್ದಾರಿಯುತ ತನಿಖಾಧಿಕಾರಿಯಾದ ನೀವು ಆರೋಪಿತರ ವಿರುದ್ಧ ಆರೋಪ ರುಜುವಾತು ಪಡಿಸಲು ಪೂರಕವಾದ ಸಾಕ್ಷಿಯನ್ನು ಸಂಗ್ರಹಿಸದೇ ನಿಮ್ಮ ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ, ಬೇಜವಾಬ್ದಾರಿತನ ಹಾಗೂ ಕರ್ತವ್ಯಲೋಪವೆಸಗಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಪೊಲೀಸ್ ಆಯುಕ್ತರು, ಬೆಂಗಳೂರು ನಗರ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 26-11-2010ರ ಆದೇಶದಲ್ಲಿ ಅರ್ಜಿದಾರರ ವಾರ್ಷಿಕ ವೇತನ ಬಡ್ತಿಯನ್ನು ಮುಂದಿನ ವಾರ್ಷಿಕ ವೇತನ ಬಡ್ತಿಯ ಮೇಲೆ ದಕ್ಕೆಯಾಗದಂತೆ ಎರಡು ವರ್ಷ ಕಾಲ ಮುಂದೂಡಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಡಿ.ಜಿ. ಮತ್ತು ಐ.ಜಿ.ಪಿ., ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 15-5-2011ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತೆ,

ಬೇಜವಾಬ್ದಾರಿತನ ಹಾಗೂ ಕರ್ತವ್ಯಲೋಪವೆಸಗಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 111 ಪೊಸಿಅ 2011 ಬೆಂಗಳೂರು, ದಿನಾಂಕ: 16–10–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಹೆಚ್.ಎಸ್. ರಾಮಲಿಂಗೇಗೌಡ, ಪಿ.ಐ., ಸಿಟಿ ಮಾರ್ಕೆಟ್ ಪೊಲೀಸ್ ಠಾಣೆ, ಬೆಂಗಳೂರು ನಗರ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

PR 31

## ಒಳಾಡಳಿತ ಸಚಿವಾಲಯ

**ವಿಷಯ:** ಶ್ರೀ ಸಿ.ಪಿ. ರಾಜು, ಮಾಜಿ ಪಿ.ಸಿ.–8578, ಕೆಂಗೇರಿ ಪೊಲೀಸ್ ಠಾಣೆ, ಬೆಂಗಳೂರು ನಗರ, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**
1. ಶಿಸ್ತು ಪ್ರಾಧಿಕಾರ ಹಾಗೂ ಉಪ ಪೊಲೀಸ್ ಆಯುಕ್ತರು, ಪಶ್ಚಿಮ ವಿಭಾಗ ಬೆಂಗಳೂರು ನಗರ, ಇವರ ಆದೇಶ ಸಂಖ್ಯೆ: 10/ಆರ್–6/ಡಿಸಿಪಿ/ಪ/2010 ದಿನಾಂಕ: 16–03–2011
2. ಮೇಲ್ಮನವಿ ಪ್ರಾಧಿಕಾರ ಹಾಗೂ ಆಡಿಷನಲ್ ಪೊಲೀಸ್ ಆಯುಕ್ತರು, (ಆಡಳಿತ) ಬೆಂಗಳೂರು, ಇವರ ಆದೇಶ ಸಂಖ್ಯೆ: 20/ಅಪೀಲು–1/2011 ದಿನಾಂಕ: 26–6–2011
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 20–9–2011
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)45/2011–12 ದಿನಾಂಕ: 23–01–2012

**ಪ್ರಸ್ತಾವನೆ:**

ಶ್ರೀ ಸಿ.ಪಿ. ರಾಜು, ಇವರು ಬೆಂಗಳೂರಿನ ಕೆಂಗೇರಿ ಪೊಲೀಸ್ ಠಾಣೆಯಲ್ಲಿ ಪೊಲೀಸ್ ಕಾನ್ಸ್‌ಟೇಬಲ್ ಆಗಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯಕ್ಕೆ ಅನಧಿಕೃತವಾಗಿ ಗೈರು ಹಾಜರಾದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು, 1965ರ ನಿಯಮ 6 ರಡಿ ಇಲಾಖಾ ವಿಚಾರಣೆಗೆ ಆದೇಶಿಸಿ, ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

> "ಶ್ರೀ ಸಿ.ಪಿ. ರಾಜು, ಎಪಿಸಿ/ಪಿಸಿ.8578, ಕೆಂಗೇರಿ ಪೊಲೀಸ್ ಠಾಣೆ, ಆದ ನೀವು ಯಾವುದೇ ಮುನ್ಸೂಚನೆ ನೀಡದೇ ಹಾಗೂ ಯಾವುದೇ ರಜೆಯನ್ನು ಮಂಜೂರು ಮಾಡಿಸಿಕೊಳ್ಳದೆ, ಈಗ್ಗೆ 9 ಬಾರಿ ವಿವಿಧ ಅವಧಿಗಳಿಗೆ ಒಟ್ಟು 514 ದಿನಗಳಿಗೂ ಹೆಚ್ಚು ದಿನಗಳ ಕಾಲ ಅನಧಿಕೃತ ಗೈರುಹಾಜರಾಗಿರುತ್ತೀರಿ, ಇದು ನೀವು ಒಬ್ಬ ಹವ್ಯಾಸಿ ಗೈರುಹಾಜರಿವುಳ್ಳ ಅಸಾಮಿಯೆಂದು ಹಾಗೂ ನೀವು ವೃತ್ತಿಯಲ್ಲಿ ಆಸಕ್ತಿಯನ್ನು ಕಳೆದುಕೊಂಡಿರುವುದು ಮೇಲ್ನೋಟಕ್ಕೆ ಕಂಡು ಬಂದಿರುತ್ತೆ."

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ ಸಾಬೀತಾಗಿದೆ ಎಂದು ಸಲ್ಲಿಸಿದ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಉಪ ಪೊಲೀಸ್ ಆಯುಕ್ತರು, ಪಶ್ಚಿಮ ವಿಭಾಗ ಬೆಂಗಳೂರು ನಗರ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 16–03–2011ರ ಆದೇಶದಲ್ಲಿ ಅರ್ಜಿದಾರರನ್ನು ಸೇವೆಯಿಂದ ವಜಾಗೊಳಿಸಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಆಡಿಷನಲ್ ಪೊಲೀಸ್ ಆಯುಕ್ತರು, (ಆಡಳಿತ) ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 26–6–2011ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ಇಲಾಖಾ ವಿಚಾರಣೆ ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ ಕರ್ತವ್ಯದಲ್ಲಿ ಅನಧಿಕೃತವಾಗಿ ಗೈರು ಹಾಜರಾಗಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 104 ಪೊಸಿಅ 2011 ಬೆಂಗಳೂರು, ದಿನಾಂಕ: 16–10–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಸಿ.ಪಿ. ರಾಜು, ಮಾಜಿ ಪಿ.ಸಿ.–8578, ಕೆಂಗೇರಿ ಪೊಲೀಸ್ ಠಾಣೆ, ಬೆಂಗಳೂರು ನಗರ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

PR 32

**ಒಳಾಡಳಿತ ಸಚಿವಾಲಯ**

**ವಿಷಯ:** ಶ್ರೀ ಎಂ.ಬಿ. ನಿಂಗೇಗೌಡ, ಮಾಜಿ ಎ.ಹೆಚ್.ಸಿ.–63 ಮತ್ತು ಶ್ರೀ ಪಿ. ರಾಘವೇಂದ್ರ, ಮಾಜಿ ಎ.ಪಿ.ಸಿ.–155, ಡಿ.ಎ.ಆರ್., ದಾವಣಗೆರೆ ಜಿಲ್ಲೆ, ಇವರುಗಳ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ದಾವಣಗೆರೆ, ಇವರ ಆದೇಶ ಸಂಖ್ಯೆ: ಸಿಬ್ಬಂದಿ(5)/ಇವಿ/9/2010 (ಓ.ಬಿ. ಸಂಖ್ಯೆ: 598/2011) ದಿನಾಂಕ: 09–5–2011
2. ಮೇಲ್ಮನವಿ ಪ್ರಾಧಿಕಾರ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರ ಆದೇಶ ಸಂಖ್ಯೆ: 21, 23/ಅಪೀಲು/ ಸಿಬ್ಬಂದಿ–2/2011–12 (ಓ.ಬಿ. ಸಂಖ್ಯೆ: 146/11–12 ದಿನಾಂಕ: 28–12–11
3. ಅರ್ಜಿದಾರರುಗಳ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 23–02–12
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)81/2011–12 ದಿನಾಂಕ: 28–5–2012

**ಪ್ರಸ್ತಾವನೆ:**

ಶ್ರೀ ಎಂ.ಬಿ. ನಿಂಗೇಗೌಡ, ಇವರು ಎ.ಹೆಚ್.ಸಿ. ಆಗಿ ಹಾಗೂ ಶ್ರೀ ಸಿ. ರಾಘವೇಂದ್ರ ಇವರು ಎ.ಪಿ.ಸಿ. ಆಗಿ ಜಿಲ್ಲಾ ಸಶಸ್ತ್ರ ಪಡೆ, ದಾವಣಗೆರೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯಲೋಪವೆಸಗಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು, 1965ರ ನಿಯಮ 6 ರಡಿ 8 ರೊಂದಿಗೆ ಜಂಟಿ ಇಲಾಖಾ ವಿಚಾರಣೆಗೆ ಆದೇಶಿಸಿ ಈ ಕೆಳಕಂಡ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

1) ದಿನಾಂಕ: 26–9–2010 ರಂದು ನಿಮ್ಮನ್ನು ದಾವಣಗೆರೆ ಬಂಧೀಖಾನೆಯಲ್ಲಿ ವಿಚಾರಣಾಧೀನ ಖೈದಿಯಾಗಿರುವ ರಮೇಶ್ ಬಿನ್ ಶಿವಮೂರ್ತಪ್ಪನನ್ನು ಸಿ.ಸಿ. ನಂ: 203/20 ರಲ್ಲಿ ಹಾಸನ ಜಿಲ್ಲೆಯ ಬೇಲೂರು ನ್ಯಾಯಾಲಯಕ್ಕೆ ಹಾಜರ್ಪಡಿಸುವ ಅತೀ ಮುಖ್ಯ ಬೆಂಗಾವಲು ಕರ್ತವ್ಯಕ್ಕೆ ನಿಯೋಜಿಸಿದ್ದು, ಅನೇಕ ಡಕಾಯಿತಿ ಕಳ್ಳತನ ಪ್ರಕರಣಗಳಲ್ಲಿ ಭಾಗಿಯಾಗಿರುವಂತಹ ವಿಚಾರಣಾಧೀನ ಖೈದಿಯ ಬೆಂಗಾವಲು ಕರ್ತವ್ಯಕ್ಕೆ ಹೆಚ್ಚಿನ ಭದ್ರತೆ ದೃಷ್ಟಿಯಿಂದ ರೈಫಲ್ ತೆಗೆದುಕೊಂಡು ಹೋಗದೇ ಕರ್ತವ್ಯಲೋಪವೆಸಗಿರುತ್ತೀರಿ.

2) ಸದರಿ ವಿಚಾರಣಾಧೀನ ಖೈದಿಯನ್ನು ನ್ಯಾಯಾಲಯಕ್ಕೆ ಹಾಜರ್ಪಡಿಸಿ ದಿನಾಂಕ: 27–9–2010 ರಂದು ವಾಪಾಸ್ ಕರೆತರುವಾಗ ಕೈಕೊಳ ಮತ್ತು ಲೀಡಿಂಗ್ ಚೈನ್ ಹಾಕದೇ, ಬೆಂಗಾವಲು ಕರ್ತವ್ಯದಲ್ಲಿದ್ದ ನೀವು ಕರ್ತವ್ಯದಲ್ಲಿ ಅತೀಯಾದ ನಿರ್ಲಕ್ಷತೆ ಮತ್ತು ಬೇಜವಾಬ್ದಾರಿತನ ತೋರಿದ್ದರಿಂದ ಸದರಿ ಅಪಾಯಕಾರಿ ಆರೋಪಿಯು ಬೀರೂರು ಸಮೀಪದ 2ನೇ ರೈಲ್ವೆಗೇಟ್ ಹತ್ತಿರ ರಾತ್ರಿ 8–00 ಗಂಟೆ ಸಮಯದಲ್ಲಿ ಮೂತ್ರ ವಿಸರ್ಜನೆಗೆಂದು ವಾಹನದಿಂದ ಕೆಳಗಿಳಿದು ತಪ್ಪಿಸಿಕೊಳ್ಳಲು ಕಾರಣಕರ್ತರಾಗಿರುತ್ತೀರಿ.

ಮೇಲ್ಕಂಡ ಆರೋಪದ ಮೇಲೆ ಜಂಟಿ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ ಸಾಬೀತಾಗಿದೆ ಎಂದು ಸಲ್ಲಿಸಿದ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ದಾವಣಗೆರೆ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 09–5–2011ರ ಆದೇಶದಲ್ಲಿ ಅರ್ಜಿದಾರರುಗಳನ್ನು ಸೇವೆಯಿಂದ ವಜಾಗೊಳಿಸಲಾಗಿದೆ, ದಿನಾಂಕ: 29–4–2010 ರಿಂದ 16–02–2011ರ ವರೆಗಿನ ಒಟ್ಟು 141 ದಿನಗಳ ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೇ ಪರಿಗಣಿಸಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 28–12–2011ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ಇಲಾಖಾ ವಿಚಾರಣೆ ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರುಗಳು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ ಕರ್ತವ್ಯದಲ್ಲಿ ಕರ್ತವ್ಯಲೋಪವೆಸಗಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 28 ಪೊಸಿಅ 2012 ಬೆಂಗಳೂರು, ದಿನಾಂಕ: 16–10–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಎಂ.ಬಿ. ನಿಂಗೇಗೌಡ, ಮಾಜಿ ಎ.ಹೆಚ್.ಸಿ.–63 ಮತ್ತು ಶ್ರೀ ಪಿ. ರಾಘವೇಂದ್ರ, ಮಾಜಿ ಎ.ಪಿ.ಸಿ.–155, ಡಿ.ಎ.ಆರ್., ದಾವಣಗೆರೆ ಜಿಲ್ಲೆ, ಇವರುಗಳ ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

PR 33

**ಒಳಾಡಳಿತ ಸಚಿವಾಲಯ**

**ವಿಷಯ:** ಶ್ರೀ ಮಲ್ಲಣ್ಣ, ಮಾಜಿ ಸಿ.ಪಿ.ಸಿ.–1036, ಸುಲೇಪೇಟೆ ಪೊಲೀಸ್ ಠಾಣೆ, ಗುಲ್ಬರ್ಗಾ ಜಿಲ್ಲೆ, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಗುಲ್ಬರ್ಗಾ, ಇವರ ಆದೇಶ ಸಂಖ್ಯೆ: ಇವಿ/64/2009 (ಓ.ಬಿ. ಸಂಖ್ಯೆ: 2403/2011) ದಿನಾಂಕ: 23–3–2011
2. ಮೇಲ್ಮನವಿ ಪ್ರಾಧಿಕಾರ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಈಶಾನ್ಯ ವಲಯ, ಗುಲ್ಬರ್ಗಾ, ಇವರ ಆದೇಶ ಸಂಖ್ಯೆ: ಅಪೀಲು/69/ಈವ/2011 (ಆ.ಪು. ಸಂಖ್ಯೆ: 443/ಈವ/2011) ದಿನಾಂಕ: 16–08–2011
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 09–9–2011
4. 'ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)43/2011–12 ದಿನಾಂಕ: 10–5–2012

**ಪ್ರಸ್ತಾವನೆ:**

ಶ್ರೀ ಮಲ್ಲಣ್ಣ, ಇವರು ಗುಲ್ಬರ್ಗಾದ ಸುಲೇಪೇಟೆ ಪೊಲೀಸ್ ಠಾಣೆಯಲ್ಲಿ ಸಿ.ಪಿ.ಸಿ. ಆಗಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯಕ್ಕೆ ಅನಧಿಕೃತವಾಗಿ ಗೈರುಹಾಜರಾಗಿ ಬೇಜವಾಬ್ದಾರಿತನ ಹಾಗೂ ಅಶಿಸ್ತು ಪ್ರದರ್ಶಿಸಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು 1965ರ ನಿಯಮ 6ರಡಿ ಇಲಾಖಾ ವಿಚಾರಣೆಗೆ ಆದೇಶಿಸಿ, ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

"ದಿನಾಂಕ: 06–3–2009 ರಿಂದ ಇಲ್ಲಿಯವರೆಗೂ ಕರ್ತವ್ಯಕ್ಕೆ ಅನಧಿಕೃತವಾಗಿ ಗೈರುಹಾಜರಾಗಿ ಬೇಜವಾಬ್ದಾರಿತನ ಹಾಗೂ ಅಶಿಸ್ತು ಪ್ರದರ್ಶಿಸಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ ಸಾಬೀತಾಗಿದೆ ಎಂದು ಸಲ್ಲಿಸಿದ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಗುಲ್ಬರ್ಗಾ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 23–3–2011ರ ಆದೇಶದಲ್ಲಿ ಅರ್ಜಿದಾರರನ್ನು ಸೇವೆಯಿಂದ ವಜಾಗೊಳಿಸಲಾಗಿದೆ ದಿನಾಂಕ: 06–3–09 ರಿಂದ 23–3–2011ರ ವರೆಗೆ ಅನಧಿಕೃತವಾಗಿ ಗೈರುಹಾಜರಾದ ಅವಧಿಯನ್ನು ವೇತನ ರಹಿತ ರಜೆ ಎಂದು ಪರಿಗಣಿಸಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಈಶಾನ್ಯ ವಲಯ, ಗುಲ್ಬರ್ಗಾ, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 16–8–2011ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ಇಲಾಖಾ ವಿಚಾರಣೆ ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ ಕರ್ತವ್ಯದಲ್ಲಿ ಅನಧಿಕೃತವಾಗಿ ಗೈರುಹಾಜರಾಗಿ ಬೇಜವಾಬ್ದಾರಿತನ ಹಾಗೂ ಅಶಿಸ್ತು ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 103 ಪೊಸಿಅ 2011 ಬೆಂಗಳೂರು, ದಿನಾಂಕ: 25–10–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಮಲ್ಲಣ್ಣ, ಮಾಜಿ ಸಿ.ಪಿ.ಸಿ.–1036, ಸುಲೇಪೇಟೆ ಪೊಲೀಸ್ ಠಾಣೆ, ಗುಲ್ಬರ್ಗಾ ಜಿಲ್ಲೆ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

PR 34

**ಒಳಾಡಳಿತ ಸಚಿವಾಲಯ**

**ವಿಷಯ:** ಶ್ರೀ ಎಂ. ರವಿ ಸಿ.ಪಿ.ಸಿ.–1424, ಕುಂಸಿ ಪೊಲೀಸ್ ಠಾಣೆ, ಹಾಲಿ ಭದ್ರಾವತಿ ಗ್ರಾಮಾಂತರ ಪೊಲೀಸ್ ಠಾಣೆ, ಶಿವಮೊಗ್ಗ ಜಿಲ್ಲೆ, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಶಿವಮೊಗ್ಗ ಜಿಲ್ಲೆ, ಇವರ ಆದೇಶ ಸಂಖ್ಯೆ: ಸಿಬ್ಬಂದಿ(5)/ಶಿಕ್ಷೆ/66/2010 (ಓ.ಬಿ. ಸಂಖ್ಯೆ: 142/2011) ದಿನಾಂಕ: 17–3–2011
2. ಮೇಲ್ಮನವಿ ಪ್ರಾಧಿಕಾರ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರ ಆದೇಶ ಸಂಖ್ಯೆ: 26/ಅಪೀಲು/ಸಿಬ್ಬಂದಿ–2/2011–12 (ಓ.ಬಿ. ಸಂಖ್ಯೆ: 104/2011–12) ದಿನಾಂಕ: 03–9–2011
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 23–02–2012
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)79/2011–12 ದಿನಾಂಕ: 07–5–2012

**ಪ್ರಸ್ತಾವನೆ:**

ಶ್ರೀ ಎಂ. ರವಿ ಸಿ.ಪಿ.ಸಿ. ಇವರು ಶಿವಮೊಗ್ಗ ಜಿಲ್ಲೆ ಕುಂಸಿ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತನ ಹಾಗೂ ದುರ್ನಡತೆ ಪ್ರದರ್ಶಿಸಿದ ಕಾರಣದ ಮೇಲೆ ಇವರ ವಿರುದ್ದ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು, 1965ರ ನಿಯಮ 7 ರಡಿ ಈ ಕೆಳಕಂಡ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

"ಶ್ರೀ ರವಿ ಎಂ. ಸಿಪಿಸಿ 1424, ಕುಂಸಿ ಪೊಲೀಸ್ ಠಾಣೆ ಆದ ನೀವು ದಿನಾಂಕ: 22–4–10 ರಂದು ಬೆಳಿಗ್ಗೆ ನಾರಾಯಣಪುರ ಗ್ರಾಮಸ್ಥರೊಂದಿಗೆ ಅಸಭ್ಯವಾಗಿ ವರ್ತಿಸಿ, ಅವಾಚ್ಯ ಶಬ್ದಗಳಿಂದ ಬೈದು ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತನ ಹಾಗೂ ದುರ್ನಡತೆ ಪ್ರದರ್ಶಿಸಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಶಿವಮೊಗ್ಗ ಜಿಲ್ಲೆ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 17–3–2011ರ ಆದೇಶದಲ್ಲಿ ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ತದನಂತರದ ವಾರ್ಷಿಕ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ 2 ವರ್ಷಗಳ ಕಾಲ ಮುಂದೂಡಲಾಗಿದೆ. ದಿನಾಂಕ: 28–4–2010 ರಿಂದ 02–6–2010ರ ವರೆಗಿನ ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೆ ಪರಿಗಣಿಸಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 03–9–2011ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಕರ್ತವ್ಯದಲ್ಲಿ ತೀವ್ರ ನಿರ್ಲಕ್ಷತನ ಹಾಗೂ ದುರ್ನಡತೆ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 25 ಪೊಸಿಅ 2012 ಬೆಂಗಳೂರು, ದಿನಾಂಕ: 25–10–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಎಂ. ರವಿ ಸಿ.ಪಿ.ಸಿ.–1424, ಕುಂಸಿ ಪೊಲೀಸ್ ಠಾಣೆ, ಹಾಲಿ ಭದ್ರಾವತಿ ಗ್ರಾಮಾಂತರ ಪೊಲೀಸ್ ಠಾಣೆ, ಶಿವಮೊಗ್ಗ ಜಿಲ್ಲೆ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

PR 35

## ಒಳಾಡಳಿತ ಸಚಿವಾಲಯ

**ವಿಷಯ:** ಶ್ರೀ ದಾದಾಫೀರ್ ಹೆಚ್.ಸಿ.–3486, ಯಶವಂತಪುರ ಪೊಲೀಸ್ ಠಾಣೆ, ಬೆಂಗಳೂರು ನಗರ, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಉಪ ಪೊಲೀಸ್ ಆಯುಕ್ತರು, ಬೆಂಗಳೂರು ನಗರ, ಇವರ ಆದೇಶ ಸಂಖ್ಯೆ: 02/ಡಿಈ/ಆರ್–7/ಡಿಸಿಪಿ/ಆವಿ/11 ದಿನಾಂಕ: 24–8–2011
2. ಮೇಲ್ಮನವಿ ಪ್ರಾಧಿಕಾರ ಹಾಗೂ ಅಡಿಷನಲ್ ಪೊಲೀಸ್ ಆಯುಕ್ತರು, ಆಡಳಿತ, ಬೆಂಗಳೂರು, ಇವರ ಆದೇಶ ಸಂಖ್ಯೆ: 44/ಅಪೀಲು–1/2011 ದಿನಾಂಕ: 07–12–2011
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 13–02–2012
4. ಸಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)76/2011–12 ದಿನಾಂಕ: 07–7–2012

**ಪ್ರಸ್ತಾವನೆ:**

ಶ್ರೀ ದಾದಾಫೀರ್, ಹೆಚ್.ಸಿ. ಇವರು ಬೆಂಗಳೂರಿನ ವೈಟ್‌ಫೀಲ್ಡ್ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಅತೀವ ನಿರ್ಲಕ್ಷತೆ ಹಾಗೂ ದುರ್ನಡತೆಯನ್ನು ಪ್ರದರ್ಶಿಸಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು 1965ರ ನಿಯಮ 7ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

> " ಶ್ರೀ ದಾದಾಫೀರ್ ಹೆಚ್.ಸಿ.–3486, ಆದ ನೀವು ವೈಟ್‌ಫೀಲ್ಡ್ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ದಿನಾಂಕ: 14–01–2011 ರಂದು ಸಂಜೆ 5–00 ಗಂಟೆಗೆ ಏರ್‌ಪೋರ್ಟ್ ಉಪ ವಿಭಾಗದ ಕಛೇರಿಯಲ್ಲಿ ಉಪ ವಿಭಾಗದ ಪೊಲೀಸ್ ಠಾಣೆಗೆ ಎಲ್ಲಾ ಪೊಲೀಸ್ ಇನ್ಸ್‌ಪೆಕ್ಟರ್, ಪೊಲೀಸ್ ಸಬ್–ಇನ್ಸ್‌ಪೆಕ್ಟರ್ ಮತ್ತು ಠಾಣಾ ಬರಹಗಾರರುಗಳ ಸಭೆ ಏರ್ಪಡಿಸಿ ಅಪರಾಧ ತಡೆಗಟ್ಟುವ ಹಾಗೂ ಠಾಣಾ ಮಟ್ಟದಲ್ಲಿ ಅಧಿಕಾರಿ ಮತ್ತು ಸಿಬ್ಬಂದಿಯವರಿಗೆ ನಿಯೋಜಿಸಿರುವ ಕರ್ತವ್ಯದ ಬಗ್ಗೆ ಹಾಗೂ ಇತರೆ ಕಛೇರಿ ಆಡಳಿತ ವ್ಯವಹಾರಗಳ ಕುರಿತು ಚರ್ಚಿಸಲು ಸಭೆಯನ್ನು ನಿಗಧಿಪಡಿಸಲಾಗಿದ್ದು, ಈ ಸಭೆಗೆ ನೀವು ಅನಧಿಕೃತ ಗೈರುಹಾಜರಾಗಿ ಅತೀವ ನಿರ್ಲಕ್ಷತೆ ಹಾಗೂ ದುರ್ನಡತೆಯನ್ನು ಪ್ರದರ್ಶಿಸಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಉಪ ಪೊಲೀಸ್ ಆಯುಕ್ತರು, ಬೆಂಗಳೂರು ನಗರ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 24–8–2011ರ ಆದೇಶದಲ್ಲಿ ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ಮುಂದಿನ ವಾರ್ಷಿಕ ವೇತನ ಬಡ್ತಿಗೆ ದಕ್ಕೆಯಾಗದಂತೆ ಮೂರು ತಿಂಗಳ ಕಾಲ ಮುಂದೂಡಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಅಡಿಷನಲ್ ಪೊಲೀಸ್ ಆಯುಕ್ತರು, ಆಡಳಿತ, ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 07–12–2011ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಕರ್ತವ್ಯದಲ್ಲಿ ಅತೀವ ನಿರ್ಲಕ್ಷತೆ ಹಾಗೂ ದುರ್ನಡತೆಯನ್ನು ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 20 ಪೊಸಿಅ 2012 ಬೆಂಗಳೂರು, ದಿನಾಂಕ: 25–10–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ದಾದಾಫೀರ್ ಹೆಚ್.ಸಿ.–3486, ಯಶವಂತಪುರ ಪೊಲೀಸ್ ಠಾಣೆ, ಬೆಂಗಳೂರು ನಗರ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

PR 36

## ಒಳಾಡಳಿತ ಸಚಿವಾಲಯ

**ವಿಷಯ:** ಶ್ರೀ ಮಲ್ಲೇಶಪ್ಪ, ನಿವೃತ್ತ ಎ.ಎಸ್.ಐ., ಸೈದಾಪುರ ಪೊಲೀಸ್ ಠಾಣೆ, ಯಾದಗಿರಿ ಜಿಲ್ಲೆ, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಗುಲ್ಬರ್ಗಾ, ಇವರ ಆದೇಶ ಸಂಖ್ಯೆ: ಪಿಆರ್/75/2009 (ಓ.ಬಿ. ಸಂಖ್ಯೆ: 110/2010) ದಿನಾಂಕ: 21–06–2010
2. ಮೇಲ್ಮನವಿ ಪ್ರಾಧಿಕಾರ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಈಶಾನ್ಯ ವಲಯ, ಗುಲ್ಬರ್ಗಾ, ಇವರ ಆದೇಶ ಸಂಖ್ಯೆ: ಅಪೀಲು/72/ಈವ/2011 (ಆ.ಪು. ಸಂಖ್ಯೆ: 452/ಈವ/2011/875) ದಿನಾಂಕ: 20–08–2011
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 06–9–2011
4. 'ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)44/2011–12 ದಿನಾಂಕ: 21–6–2012

**ಪ್ರಸ್ತಾವನೆ:**

ಶ್ರೀ ಮಲ್ಲೇಶಪ್ಪ ಇವರು ಗುಲ್ಬರ್ಗಾದ ಸೈದಾಪುರ ಪೊಲೀಸ್ ಠಾಣೆಯಲ್ಲಿ ಎ.ಎಸ್.ಐ., ಆಗಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ಅತೀವ ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು 1965ರ ನಿಯಮ 7 ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಡಿಸಲಾಗಿದೆ.

**ದೋಷಾರೋಪಣೆ:–**

> " ದಿನಾಂಕ: 12–10–2008 ಸೈದಾಪುರ ಪೊಲೀಸ್ ಠಾಣೆ ಗುನ್ನೆ ಸಂ: 109/108 ನೇದ್ದರ ಪ್ರಕರಣದಲ್ಲಿ ಸರಿಯಾದ ಕಲಂ ಆಳವಡಿಸದೆ ಮತ್ತು ಮೇಲಾಧಿಕಾರಿಗಳ ಆದೇಶ ಉಲ್ಲಂಘನೆ ಮಾಡಿ ಕರ್ತವ್ಯದಲ್ಲಿ ಅತೀವ ನಿರ್ಲಕ್ಷತನ ಹಾಗೂ ಬೇಜವಾಬ್ದಾರಿತನ ತೋರಿಸಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಗುಲ್ಬರ್ಗಾ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 21–06–2010ರ ಆದೇಶದಲ್ಲಿ ಅರ್ಜಿದಾರರ ಒಂದು ವಾರ್ಷಿಕ ವೇತನ ಬಡ್ತಿಯನ್ನು ಒಂದು ವರ್ಷದ ವರೆಗೆ ಮುಂದಿನ ವಾರ್ಷಿಕ ವೇತನ ಬಡ್ತಿಯ ಮೇಲೆ ಪರಿಣಾಮ ಬೀರದಂತೆ ಮುಂದೂಡಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಈಶಾನ್ಯ ವಲಯ, ಗುಲ್ಬರ್ಗಾ, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 20–08–2011ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ ಕರ್ತವ್ಯದಲ್ಲಿ ಅತೀವ ನಿರ್ಲಕ್ಷತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 102 ಪೊಸಿಅ 2011 ಬೆಂಗಳೂರು, ದಿನಾಂಕ: 25–10–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಮಲ್ಲೇಶಪ್ಪ, ನಿವೃತ್ತ ಎ.ಎಸ್.ಐ., ಸೈದಾಪುರ ಪೊಲೀಸ್ ಠಾಣೆ, ಯಾದಗಿರಿ ಜಿಲ್ಲೆ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

**P R 37**

## ಒಳಾಡಳಿತ ಸಚಿವಾಲಯ

**ವಿಷಯ:** ಶ್ರೀ ಆರ್.ಆರ್. ಪಾಟೀಲ್, ಪಿ.ಎಸ್.ಐ., ಗಂಗಾವತಿ ಸಂಚಾರ ಪೊಲೀಸ್ ಠಾಣೆ, ಕೊಪ್ಪಳ, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಕೊಪ್ಪಳ, ಇವರ ಆದೇಶ ಸಂಖ್ಯೆ: ಸಿಬ್ಬಂದಿ–4/ಶಿಕ್ಷೆ/143/2009 (ಆ.ಪು. ಸಂಖ್ಯೆ: 1201/10) ದಿನಾಂಕ: 24–11–2010
2. ಮೇಲ್ಮನವಿ ಪ್ರಾಧಿಕಾರ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಈಶಾನ್ಯ ವಲಯ, ಗುಲ್ಬರ್ಗಾ, ಇವರ ಆದೇಶ ಸಂಖ್ಯೆ: ಅಪೀಲು/24/ಈವ/2011 (ಆ.ಪು. ಸಂಖ್ಯೆ: 482/ಈವ/2011/2996) ದಿನಾಂಕ: 08–9–2011
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 08–11–2011
4. 'ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)56/2011–12 ದಿನಾಂಕ: 15–6–2012

**ಪ್ರಸ್ತಾವನೆ:**

ಶ್ರೀ ಆರ್.ಆರ್. ಪಾಟೀಲ್, ಪಿ.ಎಸ್.ಐ., ಇವರು ಬೀದರ್‌ನ ನಗರ ಪೊಲೀಸ್ ಠಾಣೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ನಿಷ್ಕಾಳಜಿತನ, ಬೇಜವಾಬ್ದಾರಿತನ ಹಾಗೂ ಕರ್ತವ್ಯಲೋಪವೆಸಗಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು 1965ರ ನಿಯಮ 7 ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

"ನೀವು ಈ ಹಿಂದೆ ಬೀದರ ನೂತನ ಪೊಲೀಸ್ ನಗರ ಪೊಲೀಸ್ ಠಾಣೆಯಲ್ಲಿ ಪಿ.ಎಸ್.ಐ. ಅಂತಾ ಕರ್ತವ್ಯ ನಿರ್ವಹಿಸುತ್ತಿದ್ದಾಗ, ನೂತನ ನಗರ ಪೊಲೀಸ್ ಠಾಣೆ ಗುನ್ನ ನಂ. 118/06, ಕಲಂ 323, 326, 504, 506 ಸಹಿತ 34 ಐಪಿಸಿ ಪ್ರಕರಣದಲ್ಲಿ ತನಿಖಾಧಿಕಾರಿಯಾದ ನಿಮಗೆ ಮಾನ್ಯ ನ್ಯಾಯಾಲಯವು ಸಾಕ್ಷಿ ಕುರಿತು ಸಮನ್ಸ್ ಜಾರಿ ಮಾಡಿದ್ದು, ಆದರೆ ನೀವು ಮಾನ್ಯ ನ್ಯಾಯಾಲಯಕ್ಕೆ ಸಾಕ್ಷಿ ನುಡಿಯುವ ಕುರಿತು ಹಾಜರಾಗದೇ ಇರುವುದರಿಂದ ಸದರಿ ಪ್ರಕರಣವು ಖುಲಾಸೆಯಾಗಲು ಕಾರಣಕರ್ತರಾಗಿ, ನೀವು ನಿಮ್ಮ ಕರ್ತವ್ಯದಲ್ಲಿ ಅತೀವ ನಿಷ್ಕಾಳಜಿತನ, ಬೇಜವಾಬ್ದಾರಿತನ ಹಾಗೂ ಕರ್ತವ್ಯಲೋಪವೆಸಗಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಕೊಪ್ಪಳ, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 24–11–2010ರ ಆದೇಶದಲ್ಲಿ ಅರ್ಜಿದಾರರ ವಾರ್ಷಿಕ ವೇತನ ಬಡ್ತಿಯನ್ನು ಮುಂದಿನ ವಾರ್ಷಿಕ ವೇತನ ಬಡ್ತಿಗಳ ಮೇಲೆ ಪರಿಣಾಮ ಬೀರದಂತೆ 3 ತಿಂಗಳ ಕಾಲ ಮುಂದೂಡಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಈಶಾನ್ಯ ವಲಯ, ಗುಲ್ಬರ್ಗಾ, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 08–9–2011ರ ಅದೇಶದಲ್ಲಿ ಶಿಸ್ತು ಪ್ರಾಧಿಕಾರದ ದಂಡನಾದೇಶವನ್ನು ಭಾಗಶಃ ಮಾರ್ಪಡಿಸಿ ಇವರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ಮುಂದಿನ ವಾರ್ಷಿಕ ವೇತನ ಬಡ್ತಿಗಳಿಗೆ ದಕ್ಕೆಯಾಗದಂತೆ 2 ತಿಂಗಳ ಕಾಲ ಮುಂದೂಡಲಾದ ದಂಡನೆಯನ್ನು ವಿಧಿಸಿದ್ದಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಕರ್ತವ್ಯದಲ್ಲಿ ನಿಷ್ಕಾಳಜಿತನ, ಬೇಜವಾಬ್ದಾರಿತನ ಹಾಗೂ ಕರ್ತವ್ಯಲೋಪವೆಸಗಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 131 ಪೊಸಿಅ 2011 ಬೆಂಗಳೂರು, ದಿನಾಂಕ: 25–10–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಆರ್.ಆರ್. ಪಾಟೀಲ್, ಪಿ.ಎಸ್.ಐ., ಗಂಗಾವತಿ ಸಂಚಾರ ಪೊಲೀಸ್ ಠಾಣೆ, ಕೊಪ್ಪಳ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

**P R 38**

**ಒಳಾಡಳಿತ ಸಚಿವಾಲಯ**

**ವಿಷಯ:** ಶ್ರೀ ಹೆಚ್.ಎಂ. ದಿನೇಶ, ಎ.ಪಿ.ಸಿ.–1239, ಸಿ.ಎ.ಆರ್.(ಕೇಂದ್ರ) ಬೆಂಗಳೂರು ನಗರ, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**
1. ಶಿಸ್ತು ಪ್ರಾಧಿಕಾರ ಹಾಗೂ ಉಪ ಪೊಲೀಸ್ ಆಯುಕ್ತರು, ಸಿ.ಎ.ಆರ್. (ಕೇಂದ್ರ) ಬೆಂಗಳೂರು, ಇವರ ಆದೇಶ ಸಂಖ್ಯೆ: ಡಿ.ಇ./32/2003–04 ದಿನಾಂಕ: 08–3–2006
2. ಮೇಲ್ಮನವಿ ಪ್ರಾಧಿಕಾರ ಹಾಗೂ ಅಪರ ಪೊಲೀಸ್ ಕಮೀಷನರ್, ಸಿ.ಎ.ಆರ್. ಬೆಂಗಳೂರು, ಇವರ ಆದೇಶ ಸಂಖ್ಯೆ: 03/ಅಪೀಲು–2/2006 ದಿನಾಂಕ: 30–01–2008
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 09–12–2009
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)67/2009–10 ದಿನಾಂಕ: 21–5–2010

**ಪ್ರಸ್ತಾವನೆ:**

ಶ್ರೀ ಹೆಚ್.ಎಂ. ದಿನೇಶ, ಪಿ.ಸಿ., ಸಿ.ಎ.ಆರ್. ಇವರು (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ತೀವ್ರ ಅಶಿಸ್ತು, ದುರ್ನಡತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿದ ಕಾರಣದ ಮೇಲೆ ಇತರೇ ಇಬ್ಬರು ಸಿಬ್ಬಂದಿಗಳೊಂದಿಗೆ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು, 1965ರ ನಿಯಮ 6 ರಡಿ ಇಲಾಖಾ ವಿಚಾರಣೆಗೆ ಆದೇಶಿಸಿ, ಈ ಕೆಳಕಂಡ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

**ಆರೋಪ 1:** ಎ.ಪಿ.ಸಿ. 1239, ಹೆಚ್.ಎಂ.ದಿನೇಶ್ "ಸಿ" ವಿಭಾಗ, ಸಿಎಆರ್ (ಕೇಂದ್ರ) ಬೆಂಗಳೂರು ಇಲ್ಲಿ ನೀವು ಆರಕ್ಷಕ ಪೇದೆಯಾಗಿ ದಿನಾಂಕ: 15–8–1997 ರಿಂದ ಕರ್ತವ್ಯ ನಿರ್ವಹಿಸುತ್ತಿದ್ದು, ನಿಮ್ಮನ್ನು ಮಾನ್ಯ ಮಾಜಿ ಸಚಿವರಾದ ಶ್ರೀ ಅಲ್ಲಂ ವೀರಭದ್ರಪ್ಪರವರ ನಿವಾಸದ ಕಾವಲುದಳ ಕರ್ತವ್ಯಕ್ಕೆ ದಿ: 11–02–2002 ರಿಂದ ನೇಮಿಸಲಾಗಿರುತ್ತದೆ. ದಿನಾಂಕ: 11–3–2004 ರಂದು ಬೆಳಿಗ್ಗೆ 8–00 ರಿಂದ ಮಧ್ಯಾಹ್ನ 02–00 ಗಂಟೆಯವರೆಗೆ ಕಾವಲುದಳ ಕರ್ತವ್ಯವನ್ನು ನಿರ್ವಹಿಸಿದ್ದು, ನಂತರ ರಾತ್ರಿ ಕರ್ತವ್ಯಕ್ಕೆ ಹಾಜರಾಗದೇ ಗೈರುಹಾಜರಾಗಿರುತ್ತೀರಿ. ದಿನಾಂಕ: 12–3–2004 ರಂದು ಬೆಳಿಗ್ಗೆ 08–00 ರಿಂದ 02–00 ಗಂಟೆಯವರೆಗೂ ಕರ್ತವ್ಯ ನಿರ್ವಹಿಸಿ, ನಂತರ ದಿನಾಂಕ: 29–3–2004ರ ವರೆಗೆ ಕರ್ತವ್ಯಕ್ಕೆ ಅನಧಿಕೃತ ಗೈರು ಹಾಜರಾಗಿರುತ್ತೀರಿ. ನಿಮ್ಮ ಗೈರುಹಾಜರಿ ಬಗ್ಗೆ ಮೇಲಾಧಿಕಾರಿಗಳ ಅನುಮತಿಯನ್ನಾಗಲೀ, ಅಥವಾ ಗಾರ್ಡ್ ಪುಸ್ತಕದಲ್ಲಿ ನಮೂದಿಸುವುದಾಗಲೀ ಅಥವಾ ಯಾವ ಕಾರಣಕ್ಕೆ ಗೈರುಹಾಜರಾದರೆಂಬುದರ ಬಗ್ಗೆ ಸಮಜಾಯಿಷಿಯನ್ನು ಸಹ ನೀಡಿರುವುದಿಲ್ಲ. ಇದು ನಿಮ್ಮ ಕರ್ತವ್ಯದಲ್ಲಿನ ತೀವ್ರ ಅಶಿಸ್ತು, ದುರ್ನಡತೆ ಮತ್ತು ಬೇಜವಾಬ್ದಾರಿತನವನ್ನು ಎತ್ತಿ ತೋರಿಸುತ್ತದೆ.

**ಆರೋಪ–2:** ಎ.ಪಿ.ಸಿ. 1239, ಹೆಚ್.ಎಂ. ದಿನೇಶ್ "ಸಿ" ವಿಭಾಗ, ಸಿಎಆರ್ (ಕೇಂದ್ರ) ಬೆಂಗಳೂರು ಆದ ನೀವು ದಿನಾಂಕ: 11–3–2004 ರಂದು ಸಂಜೆ ಸುಮಾರು 06–30ರ ಸಮಯದಲ್ಲಿ ಬ್ಯಾಟರಾಯನಪುರ ಪೊಲೀಸ್ ಠಾಣೆಯ ಸರಹದ್ದಿನ ಮೈಸೂರು ರಸ್ತೆ, ಬಾಪೂಜಿ ನಗರ, ಮಾರುತಿ ನಗರದ 3ನೇ ಮೈನ್, 5ನೇ ಅಡ್ಡರಸ್ತೆಯಲ್ಲಿ ಹಾಗೂ ಮಾರುತಿನಗರ ಬಾಪೂಜಿನಗರಕ್ಕೆ ಹೋಗುವ ರಸ್ತೆಯಲ್ಲಿ, ಮತ್ತು ವಿಜಯನಗರ 2ನೇ ಹಂತ 4ನೇ ಅಡ್ಡರಸ್ತೆಯಲ್ಲಿ ಇರುವ ರಾಘವೇಂದ್ರ ಸಸ್ಯಾಹಾರಿ ಹೋಟೆಲ್ ಮುಂದೆ, ನಿಮ್ಮ ಕೆಲವು ಸ್ನೇಹಿತರೊಂದಿಗೆ ದೊಡ್ಡರೇವಣ್ಣ @ ರೇವಣ್ಣ, ಬಿನ್ ಜಿವನ ಹೆಗ್ಡೆ @ ಬೋರಯ್ಯ, # 23/1/, 11ನೇ ಕ್ರಾಸ್, 4ನೇ ಮೈನ್ ಬಾಪೂಜಿನಗರ, ಮೈಸೂರು ರಸ್ತೆ, ಬೆಂಗಳೂರು ರವರ ಮೇಲೆ ಹಲ್ಲೆ ಮಾಡಿದ್ದು, ಹಲ್ಲೆಗೀಡಾದ ವ್ಯಕ್ತಿ ಕೊಲೆಯಾಗಿದ್ದು, ಈ ಬಗ್ಗೆ ಬ್ಯಾಟರಾಯನಪುರ ಪೊಲೀಸ್ ಠಾಣೆ, ಬೆಂಗಳೂರು, ಮೊಕದ್ದಮೆ ಸಂಖ್ಯೆ:

145/04 ಕಲಂ 302, 201, 109 ಸಹಿತ 34 ಐಪಿಸಿ ಪ್ರಕಾರ ದಾಖಲಾಗಿರುವ ಪ್ರಕರಣದಲ್ಲಿ ನೀವು ಸಹ ಭಾಗಿಯಾಗಿರುತ್ತೀರಿ, ನೀವು ಪೊಲೀಸ್ ಇಲಾಖೆಯಲ್ಲಿ ಒಬ್ಬ ಜವಾಬ್ದಾರಿಯುತ ಆರಕ್ಷಕ ಪೇದೆಯಾಗಿದ್ದು, ಪೊಲೀಸ್ ಪೇದೆಗೆ ತರವಲ್ಲದ ರೀತಿಯಲ್ಲಿ ವರ್ತಿಸಿ ತೀವ್ರ ದುರ್ನಡತೆಯನ್ನು ಪ್ರದರ್ಶಿಸಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ ಸಾಬೀತಾಗಿದೆ ಎಂದು ಸಲ್ಲಿಸಿದ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಉಪ ಪೊಲೀಸ್ ಆಯುಕ್ತರು, ಸಿ.ಎ.ಆರ್. (ಕೇಂದ್ರ) ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ: (1)ರಲ್ಲಿ ಓದಲಾದ ದಿನಾಂಕ: 08–3–2006ರ ಆದೇಶದಲ್ಲಿ ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು 6 ತಿಂಗಳು ಕಾಲ ಮುಂದಿನ ವಾರ್ಷಿಕ ವೇತನ ಬಡ್ತಿಗಳಿಗೆ ದಕ್ಕೆಯಾಗದಂತೆ ಮುಂದೂಡಲಾಗಿದೆ. ಅನಧಿಕೃತವಾಗಿ ಗೈರುಹಾಜರಾದ ದಿನಾಂಕ: 11–3–2004 ರಿಂದ 29–3–2004ರ ವರೆಗಿನ ಅವಧಿಯನ್ನು "ಸಂಬಳರಹಿತ ರಜೆ" ಎಂದು ಹಾಗೂ ದಿನಾಂಕ: 30–3–04 ರಿಂದ 30–11–04ರ ವರೆಗಿನ ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೆ ಪರಿಗಣಿಸಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಅಪರ ಪೊಲೀಸ್ ಕಮೀಷನರ್, ಸಿ.ಎ.ಆರ್. ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 30–01–2008ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ಇಲಾಖಾ ವಿಚಾರಣೆ ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಕರ್ತವ್ಯದಲ್ಲಿ ತೀವ್ರ ಅಶಿಸ್ತು, ದುರ್ನಡತೆ ಹಾಗೂ ಬೇಜವಾಬ್ದಾರಿತನ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 214 ಪೊಸಿಅ 2009 ಬೆಂಗಳೂರು, ದಿನಾಂಕ: 05–7–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಹೆಚ್.ಎಂ. ದಿನೇಶ, ಎ.ಪಿ.ಸಿ.–1239, ಸಿ.ಎ.ಆರ್.(ಕೇಂದ್ರ) ಬೆಂಗಳೂರು ನಗರ, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

P R 39

## ಒಳಾಡಳಿತ ಸಚಿವಾಲಯ

**ವಿಷಯ:** ಶ್ರೀ ಹೆಚ್. ಲಕ್ಷ್ಮಣ, ಹೆಡ್ ಕಾನ್ಸ್‌ಟೇಬಲ್ (ನಿಸ್ತಂತು) ಡಿ.ಜಿ.ಪಿ. ನಿಯಂತ್ರಣ ಕೊಠಡಿ, ಬೆಂಗಳೂರು, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಪೊಲೀಸ್ ಅಧೀಕ್ಷಕರು (ನಿಸ್ತಂತು) ಬೆಂಗಳೂರು ಇವರ ಆದೇಶ ಸಂಖ್ಯೆ: ಇವಿ(1)ನಿ:2001–02 (ಓ.ಬಿ. ಸಂಖ್ಯೆ: 163/2001–02) ದಿನಾಂಕ: 13–3–2002
2. ಮೇಲ್ಮನವಿ ಪ್ರಾಧಿಕಾರ ಹಾಗೂ ಡೆಪ್ಯೂಟಿ ಇನ್ಸ್‌ಪೆಕ್ಟರ್ ಜನರಲ್ ಆಫ್ ಪೊಲೀಸ್, ವೈರ್‌ಲೆಸ್, ಬೆಂಗಳೂರು, ಇವರ ಹಿಂಬರಹ ಸಂಖ್ಯೆ: ಸಿಬ್ಬಂದಿ(1)/ 40/ನಿ/2009–10 ದಿನಾಂಕ: 28–6–2010
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 30–06–2011
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)27/2011–12 ದಿನಾಂಕ: 09–02–2012

**ಪ್ರಸ್ತಾವನೆ:**

ಶ್ರೀ ಹೆಚ್. ಲಕ್ಷ್ಮಣ, ಹೆಚ್.ಸಿ. (ನಿಸ್ತಂತು) ಇವರು ಬೆಂಗಳೂರಿನಲ್ಲಿನ ಕೇಂದ್ರ ಸ್ಥಾನದ ಆಡಳಿತ ಕಛೇರಿಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಸರ್ಕಾರಿ ಹಣದ ನಷ್ಟ, ಘೋರ ದುರ್ನಡತೆ ಮತ್ತು ಕರ್ತವ್ಯದಲ್ಲಿ ನಿರ್ಲಕ್ಷತೆಯ ಆರೋಪದ ಮೇಲೆ ಇವರ ವಿರುದ್ದ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು, 1965ರ ನಿಯಮ 6 ರಡಿ ಇಲಾಖಾ ವಿಚಾರಣೆಗೆ ಆದೇಶಿಸಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

"ನೀವು, ಶ್ರೀ ಲಕ್ಷ್ಮಣ, ಮುಖ್ಯಪೇದೆ (ನಿಸ್ತಂತು) ಆಡಳಿತ ಕಛೇರಿ (ನಿಸ್ತಂತು), ಕೇಂದ್ರ ಸ್ಥಾನ ಬೆಂಗಳೂರಿನಲ್ಲಿ ಕರ್ತವ್ಯ ನಿರತರಾಗಿದ್ದಾಗ ದಿನಾಂಕ: 06–6–2001 ರಂದು ರಾಜ್ಯ ಹುಜೂರ್ ಖಜಾನೆಯಿಂದ ತಂದ ನಾಲ್ಕು ಚೆಕ್‌ಗಳ ಮೊತ್ತ ರೂ. 2,04,074–00 ಗಳನ್ನು ರಿಸರ್ವ್ ಬ್ಯಾಂಕ್‌ನಿಂದ ನಗದೀಕರಿಸಿಕೊಂಡು ಬರಲು ತಿಳಿಸಲಾಗಿತ್ತು. ನಿಮಗೆ ಬ್ಯಾಂಕ್‌ಗೆ ಹೋಗುವ ಸಮಯದಲ್ಲಿ ಕರ್ತವ್ಯದಲ್ಲಿ ಇರುವ ಅಧಿಕಾರಿಗಳನ್ನು ಕರೆದುಕೊಂಡು ಹೋಗಲು ಸಹ ತಿಳಿಸಲಾಗಿತ್ತು. ಆದರೆ ಮೇಲಾಧಿಕಾರಿಗಳ ಆಜ್ಞೆ ಉಲ್ಲಂಘನೆ ಮಾಡಿ, ರಿಸರ್ವ್ ಬ್ಯಾಂಕ್‌ಗೆ ನೀವು ಒಬ್ಬರೇ ಹೋಗಿ ಸದರಿ ಹಣವನ್ನು ನಗದೀಕರಿಸಿದ ನಂತರ ಕಳೆದುಕೊಂಡಿರುತ್ತೀರಿ. ನೀವು ಒಬ್ಬ ಜವಾಬ್ದಾರಿಯುತ ಹುದ್ದೆಯಲ್ಲಿದ್ದು, ಶಿಸ್ತಿನ ಇಲಾಖೆಯ ನೌಕರನಾಗಿದ್ದು, ಶಿಸ್ತನ್ನು ಉಲ್ಲಂಘನೆ ಮಾಡಿರುವುದರಿಂದ ನಿಮ್ಮ ಮೇಲೆ ಈ ಕೆಳಗಿನಂತೆ ದೋಷಾರೋಪಣೆ ನಿಗದಿಪಡಿಸಿರುತ್ತದೆ.

1. ಸರಕಾರಿ ಹಣದ ನಷ್ಟ.

2. ಘೋರ ದುರ್ನಡತೆ ಮತ್ತು ಕರ್ತವ್ಯದಲ್ಲಿ ನಿರ್ಲಕ್ಷ್ಯತೆ."

ಮೇಲ್ಕಂಡ ಆರೋಪದ ಮೇಲೆ ಇಲಾಖಾ ವಿಚಾರಣೆ ನಡೆಸಿ, ವಿಚಾರಣಾಧಿಕಾರಿಗಳು ಆರೋಪ ಸಾಬೀತಾಗಿದೆ ಎಂದು ಸಲ್ಲಿಸಿದ ವರದಿ ಆಧಾರದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಪೊಲೀಸ್ ಅಧೀಕ್ಷಕರು (ನಿಸ್ತಂತು) ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 13–3–2002ರ ಆದೇಶದಲ್ಲಿ ಅರ್ಜಿದಾರರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ತದನಂತರದ ವಾರ್ಷಿಕ ವೇತನ ಬಡ್ತಿಗಳಿಗೆ ದಕ್ಕಯಾಗುವಂತೆ ಮೂರು ವರ್ಷಗಳ ಕಾಲ ಮುಂದೂಡಲಾಗಿದೆ. ಸದರಿಯವರು ಸರ್ಕಾರಕ್ಕೆ ಉಂಟು ಮಾಡಿರುವ ನಷ್ಟ ರೂ. 2,04,074/– ಹಣವನ್ನು ಇವರ ಮಾಸಿಕ ವೇತನದಿಂದ ಪ್ರತಿ ತಿಂಗಳು ರೂ. 2,000/– ಒಟ್ಟು ಹಣ ವಸೂಲು ಆಗುವವರೆವಿಗೂ ಹಿಡಿಯತಕ್ಕದ್ದು. ಅಮಾನತ್ತಿನ ಅವಧಿಯನ್ನು ಅಮಾನತ್ತೆಂದೆ ಪರಿಗಣಿಸಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಡೆಪ್ಯೂಟಿ ಇನ್ಸ್‌ಪೆಕ್ಟರ್ ಜನರಲ್ ಆಫ್ ಪೊಲೀಸ್, ವೈರ್‌ಲೆಸ್, ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 28–6–2010ರ ಹಿಂಬರಹದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ಇಲಾಖಾ ವಿಚಾರಣೆ ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಸರ್ಕಾರಿ ಹಣದ ನಷ್ಟ, ಘೋರ ದುರ್ನಡತೆ ಮತ್ತು ಕರ್ತವ್ಯದಲ್ಲಿ ನಿರ್ಲಕ್ಷತೆ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 73 ಪೊಸಿಅ 2011 ಬೆಂಗಳೂರು, ದಿನಾಂಕ: 05–7–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಹೆಚ್. ಲಕ್ಷ್ಮಣ, ಹೆಡ್ ಕಾನ್ಸ್‌ಟೇಬಲ್ (ನಿಸ್ತಂತು) ಡಿ.ಜಿ.ಪಿ. ನಿಯಂತ್ರಣ ಕೊಠಡಿ, ಬೆಂಗಳೂರು, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೊಲೀಸ್ ಸೇವೆಗಳು)

PR 40

**ಒಳಾಡಳಿತ ಸಚಿವಾಲಯ**

**ವಿಷಯ:** ಶ್ರೀ ಅಮೀರ್‌ಜಾನ್, ಎ.ಹೆಚ್.ಸಿ.–26, ಡಿ.ಎ.ಆರ್., ಕೆ.ಜಿ.ಎಫ್, ಇವರ ಪರಿಷ್ಕರಣ ಮೇಲ್ಮನವಿಯ ಬಗ್ಗೆ ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಕೆ.ಜಿ.ಎಫ್., ಇವರ ಆದೇಶ ಸಂಖ್ಯೆ: ಸಿಬ್ಬಂದಿ(2)/ಶಿಕ್ಷೆ/28/2010 (ಓ.ಬಿ. ಸಂಖ್ಯೆ: 86/2010) ದಿನಾಂಕ: 14–5–2010
2. ಮೇಲ್ಮನವಿ ಪ್ರಾಧಿಕಾರ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಕೇಂದ್ರ ವಲಯ, ಬೆಂಗಳೂರು, ಇವರ ಆದೇಶ ಸಂಖ್ಯೆ: ಅಪೀಲು/25/ಪನ್ನಿ/2010–11 (ಓ.ಬಿ. ಸಂಖ್ಯೆ: 156/2010–11) ದಿನಾಂಕ: 03–01–2011
3. ಅರ್ಜಿದಾರರ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 22–5–2012
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)16/2012–13 ದಿನಾಂಕ: 17–7–2012

**ಪ್ರಸ್ತಾವನೆ:**

ಶ್ರೀ ಅಮೀರ್‌ಜಾನ್, ಎ.ಹೆಚ್.ಸಿ.–26, ಡಿ.ಎ.ಆರ್., ಕೆ.ಜಿ.ಎಫ್, ಇವರು (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಘೋರ ನಿರ್ಲಕ್ಷತೆ, ಬೇಜವಾಬ್ದಾರಿತನ ಹಾಗೂ ದುರ್ನಡತೆ ಪ್ರದರ್ಶಿಸಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೋಲೀಸ್ (ಶಿಸ್ತು ನಡವಳಿ) ನಿಯಮಗಳು 1965ರ ನಿಯಮ 7ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ:–**

> " ಶ್ರೀ ಅಮೀರ್‌ಜಾನ್, ಎ.ಹೆಚ್.ಸಿ.–26, ಡಿ.ಎ.ಆರ್., ಕೆ.ಜಿ.ಎಫ್, ಆದ ನೀವು ಒಬ್ಬ ಸರ್ಕಾರಿ ನೌಕರರಾಗಿದ್ದು, ಬಿ.ಜಿ.ಎಂ.ಎಲ್. ಸಂಸ್ಥೆಗೆ ಸೇರಿದ ಜಮೀನುನೊಳಗೆ ಅಕ್ರಮವಾಗಿ ಪ್ರವೇಶಿಸಿರುವುದಿಲ್ಲದೆ, ಮೇಲಾಧಿಕಾರಿಗಳಿಂದ ಅನುಮತಿ ಪಡೆಯದೆ ಉದ್ದಟತನದಿಂದ ಅರೇಬಿ ಶಾಲೆಯನ್ನು ಪ್ರಾರಂಭಿಸಲು ಮುಂದಾಗಿ ಘೋರ ನಿರ್ಲಕ್ಷ್ಯತೆ, ಬೇಜವಾಬ್ದಾರಿ, ಅಶಿಸ್ತು ಮತ್ತು ದುರ್ನಡತೆಯನ್ನು ಪ್ರದರ್ಶಿಸಿರುತ್ತೀರಿ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೋಲೀಸ್ ಅಧೀಕ್ಷಕರು, ಕೆ.ಜಿ.ಎಫ್., ಇವರು ಮೇಲೆ ಕ್ರಮ ಸಂಖ್ಯೆ:(1)ರಲ್ಲಿ ಓದಲಾದ ದಿನಾಂಕ: 14–5–2010ರ ಆದೇಶದಲ್ಲಿ ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ಎರಡು ವರ್ಷಗಳ ಕಾಲ ಮುಂದಿನ ವಾರ್ಷಿಕ ವೇತನ ಬಡ್ತಿಗಳಿಗೆ ದಕ್ಕೆಯಾಗದಂತೆ ಮುಂದೂಡಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೋಲೀಸ್ ಮಹಾ ನಿರೀಕ್ಷಕರು, ಕೇಂದ್ರ ವಲಯ, ಬೆಂಗಳೂರು, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 03–01–2011ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಸದರಿ ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿ ಪರಿಗಣಿಸುವಂತಹ ಯಾವುದೇ ಸಮರ್ಥನೀಯ ಹೊಸ ಅಂಶಗಳು ಇರುವುದಿಲ್ಲ. ಅರ್ಜಿದಾರರು ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದು, ಕರ್ತವ್ಯದಲ್ಲಿ ಘೋರ ನಿರ್ಲಕ್ಷತೆ, ಬೇಜವಾಬ್ದಾರಿತನ ಹಾಗೂ ದುರ್ನಡತೆ ಪ್ರದರ್ಶಿಸಿರುವುದು ಸಾಬೀತಾಗಿರುತ್ತದೆ. ಆದ್ದರಿಂದ ಶಿಸ್ತು ಪ್ರಾಧಿಕಾರಿಯು ವಿಧಿಸಿರುವ ದಂಡನೆ ಆದೇಶದಲ್ಲಿ ಹಸ್ತಕ್ಷೇಪ ಮಾಡುವ ಅಗತ್ಯತೆ ಕಂಡು ಬರುತ್ತಿಲ್ಲವಾದ್ದರಿಂದ ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 58 ಪೊಸಿಅ 2012 ಬೆಂಗಳೂರು, ದಿನಾಂಕ: 16–10–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೋಲೀಸ್ ಅಧಿನಿಯಮ 1963ರ ಸೆಕ್ಷನ್ 25 ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಅಮೀರ್‌ಜಾನ್, ಎ.ಹೆಚ್.ಸಿ.–26, ಡಿ.ಎ.ಆರ್., ಕೆ.ಜಿ.ಎಫ್, ಇವರು ಸರ್ಕಾರಕ್ಕೆ ಸಲ್ಲಿಸಿದ್ದ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ತಿರಸ್ಕರಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ
**ಟಿ.ಎನ್. ರವಿಪ್ರಕಾಶ್,**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ (ಪೋಲೀಸ್ ಸೇವೆಗಳು)

**P R 126**

## ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವಾಲಯ

**ವಿಷಯ:** ಕರ್ನಾಟಕ ಆಡಳಿತ ನ್ಯಾಯ ಮಂಡಳಿಯು ಅರ್ಜಿ ಸಂಖ್ಯೆ: 5462/2008ರಲ್ಲಿ ದಿನಾಂಕ: 18.10.2012ರಂದು ನೀಡಿರುವ ಆದೇಶದನ್ವಯ ಶ್ರೀ ರಘುರಾಮ ಭಂಡಾರಿ, ಅಪರ ಔಷಧ ನಿಯಂತ್ರಕರು, ಇವರ ಬಡ್ತಿಯನ್ನು ಹಿಂಪಡೆಯುವ ಬಗ್ಗೆ.

**ಓದಲಾಗಿದೆ:** **(1)** ಸರ್ಕಾರದ ಅಧಿಸೂಚನೆ ಸಂಖ್ಯೆ: ಆಕುಕ 128 ಐಎಂಎಂ 2008 ದಿನಾಂಕ: 20–10–2008.

**(2)** ಮಾನ್ಯ ಕರ್ನಾಟಕ ಆಡಳಿತ ನ್ಯಾಯ ಮಂಡಳಿಯು ಅರ್ಜಿ ಸಂಖ್ಯೆ: 5462/2008ರಲ್ಲಿ ದಿನಾಂಕ:18.10.2012 ರಂದು ನೀಡಿದ ಆದೇಶ.

**ಪ್ರಸ್ತಾವನೆ:**

ಔಷಧ ನಿಯಂತ್ರಣ ಇಲಾಖೆಯಲ್ಲಿ ಖಾಲಿ ಇದ್ದ ಅಪರ ಔಷಧ ನಿಯಂತ್ರಕರ ಹುದ್ದೆಗೆ ಸರ್ಕಾರವು ಮೇಲೆ ಕ್ರಮಸಂಖ್ಯೆ (1)ರಲ್ಲಿ ಓದಲಾದ ಅಧಿಸೂಚನೆಯಲ್ಲಿ ಶ್ರೀ ರಘುರಾಮ ಭಂಡಾರಿ, ಉಪ ಔಷಧ ನಿಯಂತ್ರಕರು ಇವರಿಗೆ ಬಡ್ತಿ ನೀಡಿ ಅಪರ ಔಷಧ ನಿಯಂತ್ರಕರ ಹುದ್ದೆಗೆ ನೇಮಕಾತಿ ಮಾಡಿತ್ತು. ಸದರಿ ಬಡ್ತಿಯ ಆದೇಶವನ್ನು ಶ್ರೀಮತಿ ಪಾರ್ವತಿ ಆನಂದಗೌಡರ್, ಅಧೀಕ್ಷಕರು, ಔಷಧ ಪರೀಕ್ಷಾ ಪ್ರಯೋಗಾಲಯ, ಔಷಧ ನಿಯಂತ್ರಣ ಇಲಾಖೆ, ಬೆಂಗಳೂರು ಇವರು, ಕರ್ನಾಟಕ ಆಡಳಿತ ನ್ಯಾಯ ಮಂಡಳಿಯಲ್ಲಿ 5462/2008ನೇ ಸಂಖ್ಯೆಯ ಅರ್ಜಿಯನ್ನು ದಾಖಲಿಸಿ ಪ್ರಶ್ನಿಸಿದ್ದರು. ಮಾನ್ಯ ಕರ್ನಾಟಕ ಆಡಳಿತ ನ್ಯಾಯ ಮಂಡಳಿಯು ಸದರಿ ಅರ್ಜಿಯ ಬಗ್ಗೆ ದಿನಾಂಕ: 18.10.2012ರಂದು ಈ ಕೆಳಕಂಡಂತೆ ತೀರ್ಪು ನೀಡಿರುತ್ತದೆ.

" 13. in the result and for the reasons stated above, we pass the following:

i) The application is allowed and the promotion of the respondent No.2 to the cadre of Additional Drugs Controller made in notification No: ಆಕುಕ 128 ಐಎಂಎಂ 2008 dated 20.10.2008 (Annexure-A8) is quashed;

ii) However, the respondent No. 2 is not liable to refund the salary he has received as the Additional Drugs Controller since he has worked in that post;

iii) We direct the respondent no.1 to form a DPC to consider the matter afresh in the light of the observations made hereinabove;

iv) The whole process for promotion shall be completed within three months from today and the promotion order shall be issued;

v) Fresh promotion shall be effective from 20.10.2008 with all consequential benefits;

vi) Until then, the Government is at liberty to make in-charge or additional charge arrangement for the post during the intervening period.

ಮೇಲ್ಕಂಡ ಕರ್ನಾಟಕ ಆಡಳಿತ ನ್ಯಾಯ ಮಂಡಳಿಯ ಆದೇಶದಲ್ಲಿ ಶ್ರೀ ರಘುರಾಮ ಭಂಡಾರಿ, ಇವರಿಗೆ ಅಪರ ಔಷಧ ನಿಯಂತ್ರಕರ ಹುದ್ದೆಗೆ ನೀಡಿದ ಸ್ಥಾನಪನ್ನ ಪದ್ದೋನ್ನತಿಯನ್ನು ರದ್ದುಪಡಿಸಿರುವುದರಿಂದ ಅವರನ್ನು ಉಪ ಔಷಧ ನಿಯಂತ್ರಕರ ಹುದ್ದೆಯಲ್ಲಿ ಪುನರ್ ಸ್ಥಾಪಿಸಲು ಸರ್ಕಾರವು ನಿರ್ಧರಿಸಿದೆ. ಅದರಂತೆ ಈ ಆದೇಶ.

**ಸರ್ಕಾರದ ಆದೇಶ ಸಂಖ್ಯೆ: ಆಕುಕ 158 ಐಎಂಎಂ 2008 ಬೆಂಗಳೂರು, ದಿನಾಂಕ: 15.11.2012.**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ಮಾನ್ಯ ಕರ್ನಾಟಕ ಆಡಳಿತ ನ್ಯಾಯ ಮಂಡಳಿಯು ಅರ್ಜಿ ಸಂಖ್ಯೆ: 5462/2008ರಲ್ಲಿ ದಿನಾಂಕ:18.10.2012ರಂದು ನೀಡಿದ ಆದೇಶದಲ್ಲಿ ಶ್ರೀ ರಘುರಾಮ ಭಂಡಾರಿ ಇವರಿಗೆ ಅಪರ ಔಷಧ ನಿಯಂತ್ರಕರ ಹುದ್ದೆಗೆ ಸ್ಥಾನಪನ್ನ ಪದೋನ್ನತಿಯನ್ನು ನೀಡಿದ ದಿನಾಂಕ: 20.10.2008ರ ಅಧಿಸೂಚನೆಯನ್ನು ರದ್ದುಪಡಿಸಿರುವುದರಿಂದ ಶ್ರೀಯುತರನ್ನು ಉಪ ಔಷಧ ನಿಯಂತ್ರಕರ ಹುದ್ದೆಯಲ್ಲಿ ಪುನರ್ ಸ್ಥಾಪಿಸಿ ಹುಬ್ಬಳ್ಳಿ–ಧಾರವಾಡ ವಲಯದಲ್ಲಿ ಖಾಲಿಯಿರುವ ಉಪ ಔಷಧ ನಿಯಂತ್ರಕರ ಹುದ್ದೆಗೆ ಮುಂದಿನ ಆದೇಶದವರೆಗೆ ಸ್ಥಳ ನಿಯುಕ್ತಿಗೊಳಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಕೆ.ಎನ್.ಹರಿಣಿಯಮ್ಮ**

ಸರ್ಕಾರದ ಅಧೀನ ಕಾರ್ಯದರ್ಶಿ

ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ (ಭಾರತೀಯ ವೈದ್ಯ ಪದ್ಧತಿ)

**PR. 223**

## COMMERCE AND INDUSTRIES SECRETARIAT

**CORRIGENDUM**

**No. CI 289 SPI 2011, dated : 19th December, 2012.**

**Sub :** Project proposal of M/s Associate Decor Ltd., to establish "MDF and Wood Related Product Unit" at Malur Industrial Area, Kolar District-reg

**Ref :** 1) Government No. : CI 289 SPI 2011, Dated : 6-11-2012.
2) Request from M/s Associate Decor Ltd., dated : 6-12-2012.

In the order portion of Government Order No. CI 289 SPI 2011, dated : 6-11-2012 in place of the words ;

a) "KIADB to acquire and allot additional 32.28 acres of land as SUC adjacent to existing industry at 4th Phase, Malur Industrial area"

Please read as ;

a) "KIADB to allot additional 32.28 acres land in addition to 15 acres already approved for allotment vide Govt. Order No. CI 289 SPI 2011, totaling 47.28 acres on SUC basis adjacent to existing industry at 4th Phase, Malur Industrial Area, Malur"

The other terms and conditions remain the same as in the G.O. read at above.

By Order and in the name of the Governor of Karnataka,

**K.R. CHANDRAMMA**

Desk Officer (Technical Cell) (I/c),

Commerce and Industries Department.

**P.R. 4**

## COMMERCE AND INDUSTRIES SECRETARIAT

**CORRIGENDUM**

**No. CI 56 SPI 2011, dated : 14th December, 2012.**

**Sub :** Project Proposal of M/s Jamkhandi Sugars Ltd., to Unit-II for "Expansion of Plant Capacity from 2500 TCD to 5000 TCD & Co-generation from 12 MW to 27 MW" at Nadi K.D. Village, Indi Taluk, Bijapur District.-reg.

**Ref :** 1. Government Order No. : CI 56 SPI 2011, Dated : 23-2-2011.
2. Request from M/s Jamakhandi Sugars Ltd., dated : 6-7-2012.

In the order portion of Government Order No. CI 56 SPI 2011, dated : 23-2-2011 in place of

| | | |
|---|---|---|
| **Water** | : | 300 KLPD from Bhima River, subject to approval of Water Resources Department |

Please read as

| | | |
|---|---|---|
| **Water** | : | **3,000 KLPD from Bhima River, subject to approval of Water Resources Department** |

The other terms and conditions remain the same as in the G.O. read at (1) above.

By Order and in the name of the Governor of Karnataka,

**K.R. CHANDRAMMA**

Desk Officer (Technical Cell) (I/c),

Commerce and Industries Department.

**P.R. 2314**

## ಇಂಧನ ಸಚಿವಾಲಯ

**ವಿಷಯ:** ಮೆ:: ಸಾಯಿ ಕೃಷ್ಣ ಹೈಡ್ರೋ ಪವರ್ ಪ್ರೈವೇಟ್ ಲಿಮಿಟೆಡ್ ಕಂಪನಿಗೆ ಹಂಚಿಕೆಯಾಗಿರುವ ತಲಾ 2 ಮೆ.ವ್ಯಾ. ಸಾಮರ್ಥ್ಯದ ಕಿರು ಜಲ ವಿದ್ಯುತ್ ಯೋಜನೆಯನ್ನು ಮೆ:: ಕಾರೆ ಪವರ್ ರಿಸೋರ್ಸ್ಸ್ ಪ್ರೈವೇಟ್ ಲಿಮಿಟೆಡ್ ಕಂಪನಿಗೆ ವರ್ಗಾಯಿಸುವ ಬಗ್ಗೆ.

**ಓದಲಾಗಿದೆ:** 1) ಸರ್ಕಾರಿ ಆದೇಶ ಸಂಖ್ಯೆ: ಇಎನ್ 348 ಎನ್‌ಸಿಇ 2010 ದಿನಾಂಕ: 16.09.2010.

2) ಸರ್ಕಾರಿ ಆದೇಶ ಸಂಖ್ಯೆ: ಇಎನ್ 346 ಎನ್‌ಸಿಇ 2010 ದಿನಾಂಕ: 25.11.2010.

3) ವ್ಯವಸ್ಥಾಪಕ ನಿರ್ದೇಶಕರು, ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತ ರವರ ಪತ್ರ ಸಂಖ್ಯೆ: ಕೆಆರ್‌ಡಿಇ/06/ಎಸ್‌ಹೆಚ್–659–660/2012–13/2894 ದಿನಾಂಕ: 05/08.11.2012.

**ಪ್ರಸ್ತಾವನೆ :–**

ಓದಲಾದ ಕ್ರಮ ಸಂಖ್ಯೆ (1) ರ ಆದೇಶದಲ್ಲಿ ಮೆ:: ಸಾಯಿ ಕೃಷ್ಣ ಹೈಡ್ರೋ ಪವರ್ ಪ್ರೈವೇಟ್ ಲಿಮಿಟೆಡ್ ಇವರಿಗೆ ರಾಯಚೂರು ಜಿಲ್ಲೆಯ ಲಿಂಗಸಗೂರು ತಾಲ್ಲೂಕಿನ ಹಂಚಿನಾಲ್ ಗ್ರಾಮದ ಬಳಿ ಕೃಷ್ಣ ನದಿಗೆ ಅಡ್ಡಲಾಗಿ 2.00 ಮೆಗಾ ವ್ಯಾಟ್ ಸಾಮರ್ಥ್ಯದ ಕಿರು ಜಲ ವಿದ್ಯುತ್ ಯೋಜನೆಯನ್ನು (Weir **Latitude**: 16°12'15'' **Longitude**: 76°27'26'' Power House-**Latitude**: 16°14'52'' **Longitude**: 76°28'04'') ಕೆಲವು ನಿಬಂಧನೆಗೊಳಪಟ್ಟು ಹಂಚಿಕೆ ಮಾಡಿ ಆದೇಶಿಸಲಾಗಿತ್ತು.

ಓದಲಾದ ಕ್ರಮ ಸಂಖ್ಯೆ (2) ರ ಆದೇಶದಲ್ಲಿ ಮೆ:: ಸಾಯಿ ಕೃಷ್ಣ ಹೈಡ್ರೋ ಪವರ್ ಪ್ರೈವೇಟ್ ಲಿಮಿಟೆಡ್ ಇವರಿಗೆ ರಾಯಚೂರು ಜಿಲ್ಲೆಯ ಲಿಂಗಸುಗುರು ತಾಲ್ಲೂಕಿನ ಗೊನವಟಾಲ್ ಗ್ರಾಮದ ಬಳಿ ಕೃಷ್ಣ ನದಿಗೆ ಅಡ್ಡಲಾಗಿ 2.00 ಮೆಗಾ ವ್ಯಾಟ್ ಸಾಮರ್ಥ್ಯದ ಕಿರು ಜಲ ವಿದ್ಯುತ್ ಯೋಜನೆಯನ್ನು (Weir Latitude: 16°16'53'' Longitude: 76°30'11'' Power House-Latitude: 16°17'15'' Longitude: 76°31'04'') ಕೆಲವು ನಿಬಂಧನೆಗೊಳಪಟ್ಟು ಹಂಚಿಕೆ ಮಾಡಿ ಆದೇಶಿಸಲಾಗಿತ್ತು.

ಓದಲಾದ ಕ್ರಮ ಸಂಖ್ಯೆ (3) ರ ಪತ್ರದಲ್ಲಿ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ ವ್ಯವಸ್ಥಾಪಕ ನಿರ್ದೇಶಕರು ಮೆ:: ಸಾಯಿ ಕೃಷ್ಣ ಪವರ್ ಪ್ರೈವೇಟ್ ಲಿಮಿಟೆಡ್ ಕಂಪನಿಗೆ ರಾಯಚೂರು ಜಿಲ್ಲೆಯ ಲಿಂಗಸಗೂರು ತಾಲ್ಲೂಕಿನ ಹಂಚಿನಾಲ್ ಗ್ರಾಮದ ಬಳಿ ಕೃಷ್ಣ ನದಿಗೆ ಅಡ್ಡಲಾಗಿ ಹಂಚಿಕೆಯಾಗಿರುವ 2.00 ಮೆಗಾ ವ್ಯಾಟ್ ಸಾಮರ್ಥ್ಯದ ಕಿರು ಜಲ ವಿದ್ಯುತ್ ಯೋಜನೆ ಹಾಗೂ ಅದೇ ಜಿಲ್ಲೆ ಮತ್ತು ತಾಲ್ಲೂಕಿನ ಗೊನವಟಾಲ್ ಗ್ರಾಮದ ಬಳಿ ಕೃಷ್ಣ ನದಿಗೆ ಅಡ್ಡಲಾಗಿ ಹಂಚಿಕೆಯಾಗಿರುವ 2.00 ಮೆಗಾ ವ್ಯಾಟ್ ಸಾಮರ್ಥ್ಯದ ಕಿರು ಜಲ ವಿದ್ಯುತ್ ಯೋಜನೆಯನ್ನು ಮೆ: ಕಾರೆ ಪವರ್ ರಿಸೋರ್ಸ್ಸ್ ಪ್ರೈವೇಟ್ ಲಿಮಿಟೆಡ್ ಕಂಪನಿಯ ಹೆಸರಿಗೆ ವರ್ಗಾಯಿಸಲು ಅಭಿವೃದ್ಧಿದಾರರ ಕೋರಿಕೆ ಮೇರೆಗೆ ಪ್ರಸ್ತಾವನೆಯನ್ನು ಶಿಫಾರಸ್ಸು ಮಾಡಿ ಸರ್ಕಾರಕ್ಕೆ ಕಳುಹಿಸಿರುತ್ತಾರೆ.

ಸದರಿ ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ, ಈ ಕೆಳಗಿನಂತೆ ಆದೇಶಿಸಲಾಗಿದೆ :–

**ಸರ್ಕಾರಿ ಆದೇಶ ಸಂಖ್ಯೆ: ಇಎನ್ 346 ಎನ್‌ಸಿಇ 2012, ಬೆಂಗಳೂರು, ದಿನಾಂಕ: 27.12.2012.**

ಮೆ:: ಸಾಯಿ ಕೃಷ್ಣ ಹೈಡ್ರೋ ಪವರ್ ಪ್ರೈವೇಟ್ ಲಿಮಿಟೆಡ್ ಕಂಪನಿಗೆ ರಾಯಚೂರು ಜಿಲ್ಲೆಯ ಲಿಂಗಸಗೂರು ತಾಲ್ಲೂಕಿನ ಹಂಚಿನಾಲ್ ಹಾಗೂ ಗೊನವಟಾಲ್ ಗ್ರಾಮದ ಬಳಿ ಕೃಷ್ಣ ನದಿಗೆ ಅಡ್ಡಲಾಗಿ ಹಂಚಿಕೆಯಾಗಿರುವ ತಲಾ 2.00 ಮೆಗಾ ವ್ಯಾಟ್ ಸಾಮರ್ಥ್ಯದ ಕಿರು ಜಲ ವಿದ್ಯುತ್ ಯೋಜನೆಗಳನ್ನು ಈ ಕೆಳಕಂಡ ಷರತ್ತಿಗೊಳಪಟ್ಟು ಮೆ:: ಕಾರೆ ಪವರ್ ರಿಸೋರ್ಸ್ಸ್ ಪ್ರೈವೇಟ್ ಲಿಮಿಟೆಡ್ ಕಂಪನಿಗೆ ವರ್ಗಾಯಿಸಿ ಆದೇಶಿಸಿದೆ.

1) **ಮೆ : ಕಾರೆ ಪವರ್ ರಿಸೋರ್ಸ್ಸ್ ಪ್ರೈವೇಟ್ ಲಿಮಿಟೆಡ್** ಕಂಪನಿಯವರು 45 ದಿನಗಳ ಒಳಗಾಗಿ ಸರ್ಕಾರಿ ಆದೇಶ ಸಂಖ್ಯೆ ಇಎನ್ 435 ಎನ್‌ಸಿಇ 2011 ದಿನಾಂಕ 06.1.2012 ರನ್ವಯ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದೊಂದಿಗೆ ನಿಯಮಾನುಸಾರ ಒಡಂಬಡಿಕೆ ಮಾಡಿಕೊಳ್ಳತಕ್ಕದ್ದು.
2) **ಮೆ : ಕಾರೆ ಪವರ್ ರಿಸೋರ್ಸ್ಸ್ ಪ್ರೈವೇಟ್ ಲಿಮಿಟೆಡ್** ಕಂಪನಿಯವರು ಈ ಯೋಜನೆಯ ವರ್ಗಾವಣೆಗೆ ಸಂಬಂಧಿಸಿದಂತೆ ಸರ್ಕಾರದ ಆದೇಶಾನುಸಾರ ಅವಶ್ಯವಿರುವ ವರ್ಗಾವಣೆ ಶುಲ್ಕವನ್ನು ಪಾವತಿಸತಕ್ಕದ್ದು.
3) **ಮೆ : ಕಾರೆ ಪವರ್ ರಿಸೋರ್ಸ್ಸ್ ಪ್ರೈವೇಟ್ ಲಿಮಿಟೆಡ್** ಕಂಪನಿಯವರು ವಿದ್ಯುತ್ ಖರೀದಿ ಒಪ್ಪಂದವನ್ನು ಸಂಬಂಧಿಸಿದ ವಿದ್ಯುತ್ ಸರಬರಾಜು ಕಂಪನಿಯೊಂದಿಗೆ ಮಾಡಿಕೊಳ್ಳತಕ್ಕದ್ದು.
4) ಸದರಿ ಯೋಜನೆಯನ್ನು ಸರ್ಕಾರಿ ಆದೇಶ ಸಂಖ್ಯೆ: ಇಎನ್ 348 ಎನ್‌ಸಿಇ 2010 ದಿನಾಂಕ: 16.09.2010 ಮತ್ತು ಸರ್ಕಾರಿ ಆದೇಶ ಸಂಖ್ಯೆ: ಇಎನ್ 346 ಎನ್‌ಸಿಇ 2010 ದಿನಾಂಕ: 25.11.2010ರ ಆದೇಶಗಳಲ್ಲಿ ನಿಗದಿಪಡಿಸಿದ ಕಾಲಮಿತಿಯೊಳಗಾಗಿ ಅನುಷ್ಠಾನಗೊಳಿಸತಕ್ಕದ್ದು.
5) ಸದರಿ ಆದೇಶವನ್ನು ರದ್ದು ಪಡಿಸುವುದು/ಮಾರ್ಪಾಡು ಮಾಡುವ ಅಧಿಕಾರವನ್ನು ಸರ್ಕಾರವು ಹೊಂದಿರುತ್ತದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,
**ಕೌಸಲ್ಯಾ**
ಸರ್ಕಾರದ ಅಧೀನ ಕಾರ್ಯದರ್ಶಿ,
ಇಂಧನ ಇಲಾಖೆ.

**PR.12**

## ಇಂಧನ ಸಚಿವಾಲಯ

**ವಿಷಯ:** ಮೆ: ಶ್ರೀ ರಾಮ್ಕೋ ಬಯೋಟೆಕ್ ಕಂಪನಿಯವರು ಅನುಷ್ಠಾನಗೊಳಿಸಿರುವ 0.33 ಮೆ.ವ್ಯಾ. ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಯನ್ನು ಮೆ: ರಾಮ್ಕೋ ಇಂಡಸ್ಟ್ರೀಸ್ ಲಿಮಿಟೆಡ್ ರವರಿಗೆ ವರ್ಗಾವಣೆ ಮಾಡುವ ಬಗ್ಗೆ.

**ಓದಲಾಗಿದೆ:** 1) ಸರ್ಕಾರಿ ಆದೇಶ ಸಂಖ್ಯೆ: ಇಎನ್ 46 ಎನ್‌ಸಿಇ 2000 ದಿನಾಂಕ: 17.7.2000.

2) ಸರ್ಕಾರಿ ಆದೇಶ ಸಂಖ್ಯೆ: ಇಎನ್ 133 ಎನ್‌ಸಿಇ 2006 ದಿನಾಂಕ: 17.3.2006.

3) ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ, ವ್ಯವಸ್ಥಾಪಕ ನಿರ್ದೇಶಕರ ಪತ್ರ ಸಂಖ್ಯೆ: ಕೆಆರ್‌ಇಡಿ/08/RIL-0.33MW/Ramco Biotech/

4) 2012/2576 ದಿನಾಂಕ: 28.9.2012.

**ಪ್ರಸ್ತಾವನೆ:–**

ಮೇಲೆ ಕ್ರಮ ಸಂಖ್ಯೆ (1) ರಲ್ಲಿ ಓದಲಾದ ಸರ್ಕಾರಿ ಆದೇಶದ ಕ್ರಮ ಸಂಖ್ಯೆ (1)ರಲ್ಲಿ ಮೆ::ಎನರ್ಕಾನ್ (ಇಂಡಿಯಾ) ಲಿಮಿಟೆಡ್ ಕಂಪನಿಗೆ ಚಿತ್ರದುರ್ಗ ಜಿಲ್ಲೆಯ ಜೋಗಿಮಟ್ಟಿ ಪ್ರದೇಶದ ಗೋಪಾಲಪುರ, ಮಹಾದೇವನಕಟ್ಟೆ ಮತ್ತು ಹೊರಕೆರೆದೇವರಪುರ ಇಲ್ಲಿ 81.60 ಮೆ.ವ್ಯಾ ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಯನ್ನು ಮಂಜೂರು ಮಾಡಿ ಆದೇಶಿಸಲಾಗಿತ್ತು.

ಮೇಲೆ ಕ್ರಮ ಸಂಖ್ಯೆ (2) ರಲ್ಲಿ ಓದಲಾದ ಸರ್ಕಾರಿ ಆದೇಶದಲ್ಲಿ ಮೆ::ಎನರ್ಕಾನ್ (ಇಂಡಿಯಾ) ಲಿಮಿಟೆಡ್ ಕಂಪನಿಗೆ ಚಿತ್ರದುರ್ಗ ಜಿಲ್ಲೆಯ ವಿವಿಧ ಪ್ರದೇಶಗಳಲ್ಲಿ ಹಂಚಿಕೆಯಾಗಿದ್ದ 81.60 ಮೆ.ವ್ಯಾ ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಯಿಂದ ಚಿತ್ರದುರ್ಗ ಜಿಲ್ಲೆಯ ಹೊಸದುರ್ಗ ತಾಲ್ಲೂಕಿನ ಜನಕಲ್ಲು ಗ್ರಾಮದಲ್ಲಿನ 0.33 ಮೆ.ವ್ಯಾ. ಸಾಮರ್ಥ್ಯವನ್ನು ಮೆ: ಶ್ರೀ ರಾಮ್ಕೋ ಬಯೋಟೆಕ್ ಇವರಿಗೆ ವರ್ಗಾವಣೆ ಮಾಡಿ ಆದೇಶಿಸಲಾಗಿತ್ತು.

ಮೇಲೆ ಓದಲಾದ (3)ರ ಪತ್ರದಲ್ಲಿ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ ವ್ಯವಸ್ಥಾಪಕ ನಿರ್ದೇಶಕರು ಮೆ: ಶ್ರೀ ರಾಮ್ಕೋ ಬಯೋಟೆಕ್ ಕಂಪನಿಯವರಿಗೆ ಚಿತ್ರದುರ್ಗ ಜಿಲ್ಲೆಯ ಹೊಸದುರ್ಗ ತಾಲ್ಲೂಕಿನ ಜನಕಲ್ ಗ್ರಾಮದಲ್ಲಿ ಮಂಜೂರಾಗಿದ್ದ 0.33 ಮೆ.ವ್ಯಾ ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಯು ದಿನಾಂಕ 29.03.2006ರಲ್ಲಿ ಅನುಷ್ಠಾನಗೊಂಡಿರುವುದಾಗಿ ತಿಳಿಸುತ್ತಾ, ಸದರಿ ಸಾಮರ್ಥ್ಯವನ್ನು ಮೆ: ರಾಮ್ಕೋ ಇಂಡಸ್ಟ್ರೀಸ್ ಲಿಮಿಟೆಡ್ ರವರಿಗೆ ವರ್ಗಾಯಿಸುವಂತೆ ಶಿಫಾರಸ್ಸು ಮಾಡಿರುತ್ತಾರೆ ಹಾಗೂ ಉತ್ಪಾದನೆ ಆಗುವ ವಿದ್ಯುತ್ತನ್ನು ವೀಲಿಂಗ್ ಮತ್ತು ಬ್ಯಾಂಕಿಂಗ್ ಮುಖಾಂತರ ಪೂರಕ ವಿದ್ಯುತ್ ಖರೀದಿ ಒಪ್ಪಂದ ಮಾಡಿಕೊಳ್ಳುವುದಾಗಿ ಮತ್ತು ಸದರಿ ಯೋಜನೆಯು ಸರ್ವೆ ಸಂಖ್ಯೆ 256ರಲ್ಲಿದ್ದು, 0.462 ಹೆಕ್ಟೇರ್ ಅರಣ್ಯ ಇಲಾಖೆಗೆ ಸೇರಿದ ಜಮೀನಿನಲ್ಲಿರುತ್ತದೆ ಎಂದು ವರದಿ ಮಾಡಿರುತ್ತಾರೆ.

ಸದರಿ ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ, ಈ ಕೆಳಗಿನಂತೆ ಆದೇಶಿಸಲಾಗಿದೆ:–

**ಸರ್ಕಾರಿ ಆದೇಶ ಸಂಖ್ಯೆ: ಇಎನ್ 300 ಎನ್‌ಸಿಇ 2012, ಬೆಂಗಳೂರು, ದಿನಾಂಕ: 25.10.2012.**

ಮೆ :: ಶ್ರೀ ರಾಮ್ಕೋ ಬಯೋಟೆಕ್ ಕಂಪನಿಯವರಿಗೆ ಚಿತ್ರದುರ್ಗ ಜಿಲ್ಲೆಯ ಹೊಸದುರ್ಗ ತಾಲ್ಲೂಕಿನ ಜನಕಲ್ ಗ್ರಾಮದಲ್ಲಿ ಮಂಜೂರಾಗಿ ಅನುಷ್ಠಾನಗೊಂಡಿರುವ 0.33 ಮೆ.ವ್ಯಾ ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಯನ್ನು ಮೆ: ರಾಮ್ಕೋ ಇಂಡಸ್ಟ್ರೀಸ್ ಲಿಮಿಟೆಡ್ ರವರಿಗೆ ಈ ಕೆಳಕಂಡ ಷರತ್ತಿಗೊಳಪಟ್ಟು **ವರ್ಗಾಯಿಸಲಾಗಿದೆ** :

1 **ಮೆ:: ರಾಮ್ಕೋ ಇಂಡಸ್ಟ್ರೀಸ್ ಲಿಮಿಟೆಡ್** ರವರು 45 ದಿನಗಳ ಒಳಗಾಗಿ ಸರ್ಕಾರಿ ಆದೇಶ ಸಂಖ್ಯೆ ಇಎನ್ 435 ಎನ್‌ಸಿಇ 2011 ದಿನಾಂಕ 06.1.2012 ರನ್ವಯ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದೊಂದಿಗೆ ನಿಯಮಾನುಸಾರ ಒಡಂಬಡಿಕೆ ಮಾಡಿಕೊಳ್ಳತಕ್ಕದ್ದು.

2 **ಮೆ:: ರಾಮ್ಕೋ ಇಂಡಸ್ಟ್ರೀಸ್ ಲಿಮಿಟೆಡ್** ರವರು ಸಂಬಂಧಿಸಿದ ಎಸ್ಕಾಂ/ಕೆಪಿಟಿಸಿಎಲ್‌ನೊಂದಿಗೆ ನೀತಿ ನಿಯಮಾನುಸಾರ ವೀಲಿಂಗ್ ಮತ್ತು ಬ್ಯಾಂಕಿಂಗ್‌ಗೆ ಸಂಬಂಧಿಸಿದಂತೆ ಪೂರಕ ವಿದ್ಯುತ್ ಖರೀದಿ ಒಪ್ಪಂದ ಮಾಡಿಕೊಳ್ಳತಕ್ಕದ್ದು.

3 ಸದರಿ ಆದೇಶವನ್ನು ರದ್ದು ಪಡಿಸುವುದು/ಮಾರ್ಪಾಡು ಮಾಡುವ ಅಧಿಕಾರವನ್ನು ಸರ್ಕಾರವು ಹೊಂದಿರುತ್ತದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,
**ಕೌಸಲ್ಯಾ**
ಸರ್ಕಾರದ ಅಧೀನ ಕಾರ್ಯದರ್ಶಿ,
ಇಂಧನ ಇಲಾಖೆ.

PR.2188

## ಇಂಧನ ಸಚಿವಾಲಯ

**ವಿಷಯ:** ಮೆ:: ಗಿರಿರಾಜ್ ಎಂಟರ್‌ಪ್ರೈಸಸ್ ಕಂಪನಿಯವರಿಗೆ ಮಂಜೂರಾಗಿರುವ 2.1 ಮೆ.ವ್ಯಾ. ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಯ ಅನುಷ್ಠಾನಕ್ಕೆ ಕಾಲಾವಕಾಶ ವಿಸ್ತರಿಸುವ ಬಗ್ಗೆ.

**ಓದಲಾಗಿದೆ:** 1) ಸರ್ಕಾರಿ ಆದೇಶ ಸಂಖ್ಯೆ: ಇಎನ್ 128 ಎನ್‌ಸಿಇ 2012 ದಿನಾಂಕ: 30.7.2012.

2) ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ, ವ್ಯವಸ್ಥಾಪಕ ನಿರ್ದೇಶಕರ ಪತ್ರಗಳ ಸಂಖ್ಯೆ: KRED/08/Abletec/GE-2.1MW/HMM/2012/ 2506 ದಿನಾಂಕ: 14.9.2012 ಮತ್ತು KRED/08/Abletec/GE-2.1MW/HMM/ 2012/2580 ದಿನಾಂಕ: 28.9.2012.

**ಪ್ರಸ್ತಾವನೆ:–**

ಮೇಲೆ ಓದಲಾದ (1)ರ ಸರ್ಕಾರಿ ಆದೇಶದಲ್ಲಿ ಮೆ : ಏಬಲ್‌ಟೆಕ್ ಎಲೆಕ್ಟ್ರೋ ಇಂಜಿನೀಯರ್ಸ್ (ಪ್ರೈ) ಲಿಮಿಟೆಡ್ ಕಂಪನಿಯವರಿಗೆ ಹಾವೇರಿ ಜಿಲ್ಲೆಯಲ್ಲಿ ಅನುಷ್ಠಾನ ಮಾಡಲು ಅನುಮತಿಸಿರುವ 5.00 ಮೆ.ವ್ಯಾ ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಯಿಂದ 2.1 ಮೆ.ವ್ಯಾ. ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಯನ್ನು ಮೆ:: ಗಿರಿರಾಜ್ ಎಂಟರ್‌ಪ್ರೈಸಸ್ ಕಂಪನಿಯವರಿಗೆ ಈ ಕೆಳಗಿನ ಶೆಡ್ಯೂಲ್‌ನಲ್ಲಿ ವಿವರಿಸಿರುವಂತೆ ಹಾಗೂ ಯೋಜನೆಯನ್ನು ದಿನಾಂಕ 30.8.2012ರೊಳಗಾಗಿ ಅನುಷ್ಠಾನಗೊಳಿಸತಕ್ಕದ್ದೆಂಬ ಷರತ್ತಿಗೊಳಪಟ್ಟು ವರ್ಗಾಯಿಸಿ ಆದೇಶಿಸಲಾಗಿತ್ತು.

| Village Name | Taluk & District | MW | Land survey number | Land Sy. No | Extent in land | WTG Location No. | Latitude, Longitude and Ridge peaks |
|---|---|---|---|---|---|---|---|
| Aladhgere | Hirkerur / Haveri | 2.1 | 27 | 1 No | 2 Acres per WTG | RAN-100 | **Latitude**: 14°33'01.0"- N<br>**Longitude**:75°28'11.8"- E<br>**Ridge peaks:** 665m |

ಮೇಲೆ ಓದಲಾದ (2)ರ ದಿನಾಂಕ 14.9.2012ರ ಪತ್ರದಲ್ಲಿ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ ವ್ಯವಸ್ಥಾಪಕ ನಿರ್ದೇಶಕರು ಮೆ:: ಗಿರಿರಾಜ್ ಎಂಟರ್‌ಪ್ರೈಸಸ್ ಕಂಪನಿಯವರಿಗೆ ಹಾವೇರಿ ಜಿಲ್ಲೆಯಲ್ಲಿ ಮಂಜೂರಾಗಿರುವ 2.1 ಮೆ.ವ್ಯಾ ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಯ ಅನುಷ್ಠಾನಕ್ಕೆ ನೀಡಿರುವ ಕಾಲಾವಕಾಶವು ದಿನಾಂಕ 30.8.2012ಕ್ಕೆ ಮುಕ್ತಾಯಗೊಂಡಿದ್ದು, ಕರ್ನಾಟಕ ವಿದ್ಯುತ್ ಪ್ರಸರಣ ನಿಗಮ ನಿಯಮಿತದಿಂದ Interconnection approval ಬರಲು ಆಗಿರುವ ವಿಳಂಬದಿಂದ ಯೋಜನೆಯನ್ನು ನಿಗಧಿತ ಅವಧಿಯೊಳಗಾಗಿ ಅನುಷ್ಠಾನಗೊಳಿಸಲು ಸಾಧ್ಯವಾಗದ ಕಾರಣ ಯೋಜನೆಯ ಅನುಷ್ಠಾನಕ್ಕೆ ದಿನಾಂಕ 15.10.2012ರವರೆಗೆ ಕಾಲಾವಕಾಶವನ್ನು ವಿಸ್ತರಿಸುವಂತೆ ಅಭಿವೃದ್ಧಿದಾರರ ಕೋರಿಕೆ ಮೇರೆಗೆ ಶಿಫಾರಸ್ಸಿಸಿ ಸರ್ಕಾರಕ್ಕೆ ಪ್ರಸ್ತಾವನೆಯನ್ನು ಸಲ್ಲಿಸಿರುತ್ತಾರೆ.

ಸದರಿ ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಈ ಕೆಳಗಿನಂತೆ ಆದೇಶಿಸಲಾಗಿದೆ:–

**ಸರ್ಕಾರಿ ಆದೇಶ ಸಂಖ್ಯೆ: ಇಎನ್ 283 ಎನ್‌ಸಿಇ 2012, ಬೆಂಗಳೂರು, ದಿನಾಂಕ: 05.10.2012.**

ಮೆ:: ಗಿರಿರಾಜ್ ಎಂಟರ್‌ಪ್ರೈಸಸ್ ಕಂಪನಿಯವರಿಗೆ ಹಾವೇರಿ ಜಿಲ್ಲೆಯಲ್ಲಿ ಮಂಜೂರಾಗಿರುವ2.1 ಮೆ.ವ್ಯಾ ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಯ ಅನುಷ್ಠಾನಕ್ಕೆ ಕಾಲಾವಕಾಶವನ್ನು ದಿನಾಂಕ 31.08.2012 ರಿಂದ ದಿನಾಂಕ 15.10.2012ರವರೆಗೆ, ನಿಗಧಿತ ಕಾಲಾವಕಾಶ ಶುಲ್ಕವನ್ನು ಪಾವತಿಸತಕ್ಕದ್ದೆಂಬ ಷರತ್ತಿಗೊಳಪಟ್ಟು ವಿಸ್ತರಿಸಿ ಆದೇಶಿಸಿದೆ.

ಸದರಿ ಆದೇಶವನ್ನು ರದ್ದು ಪಡಿಸುವುದು/ಮಾರ್ಪಾಡು ಮಾಡುವ ಅಧಿಕಾರವನ್ನು ಸರ್ಕಾರವು ಹೊಂದಿರುತ್ತದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,
**ಕೌಸಲ್ಯಾ**
ಸರ್ಕಾರದ ಅಧೀನ ಕಾರ್ಯದರ್ಶಿ,
ಇಂಧನ ಇಲಾಖೆ.

**PR.2217**

## ಇಂಧನ ಸಚಿವಾಲಯ

**ವಿಷಯ:** ಮೆ॥ ಮೌಂಟ್ ಕೈಲಾಷ್ ಪವರ್ ಪ್ರಾಜೆಕ್ಟ್ ಪ್ರೈವೇಟ್ ಲಿಮಿಟೆಡ್ ಕಂಪನಿಯ ಹೆಸರನ್ನು ಮೆ : ಸೋಹಮ್ ಫಾಲ್ಗುಣಿ ರಿನ್ಯೂವೆಬಲ್ ಎನರ್ಜಿ ಪ್ರೈವೇಟ್ ಲಿಮಿಟೆಡ್ ಎಂದು ಬದಲಾಯಿಸುವ ಮತ್ತು ಸದರಿ ಕಂಪನಿಯವರ 10.5 ಮೆ.ವ್ಯಾ. ಸಾಮರ್ಥ್ಯದ ಕಿರು ಜಲ ವಿದ್ಯುತ್ ಯೋಜನೆಯ ಅನುಷ್ಠಾನಕ್ಕಾಗಿ ಕಾಲಾವಕಾಶ ವಿಸ್ತರಿಸುವ ಬಗ್ಗೆ.

**ಓದಲಾಗಿದೆ:**

1) ಸರ್ಕಾರಿ ಆದೇಶ ಸಂಖ್ಯೆ: ಇಂಇ 241 ಎನ್‌ಸಿಇ 2002 ದಿನಾಂಕ: 10.10.2002.
2) ಸರ್ಕಾರಿ ಆದೇಶ ಸಂಖ್ಯೆ: ಇಂಇ 241 ಎನ್‌ಸಿಇ 2003 ದಿನಾಂಕ: 23.10.2003.
3) ಸರ್ಕಾರಿ ಆದೇಶ ಸಂಖ್ಯೆ: ಇಂಇ 289 ಎನ್‌ಸಿಇ 2003 ದಿನಾಂಕ: 09.1.2004.
4) ಸರ್ಕಾರಿ ಆದೇಶ ಸಂಖ್ಯೆ: ಇಎನ್ 147 ಎನ್‌ಸಿಇ 2010 ದಿನಾಂಕ: 19.06.2010.
5) ಸರ್ಕಾರಿ ಆದೇಶ ಸಂಖ್ಯೆ: ಇಎನ್ 147 ಎನ್‌ಸಿಇ 2010 ದಿನಾಂಕ: 29.10.2010.
6) ವ್ಯವಸ್ಥಾಪಕ ನಿರ್ದೇಶಕರು, ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತ ಇವರ ಪತ್ರಗಳ ಸಂಖ್ಯೆ: ಕೆಆರ್‌ಇಡಿ/06/SH-100/2012–13/2330 ದಿನಾಂಕ:07/22.08.2012 ಮತ್ತು ಕೆಆರ್‌ಇಡಿ/06/SH-100/ಮಲ್ಲಿಬೆಟ್ಟು ಎಂಹೆಚ್‌ಎಸ್/2012/2828 ದಿನಾಂಕ: 02/03.11.2012.

**ಪ್ರಸ್ತಾವನೆ:–**

ಮೇಲೆ ಓದಲಾದ ಕ್ರಮ ಸಂಖ್ಯೆ (1)ರ ಆದೇಶದಲ್ಲಿ ಮೆ॥ ಮೌಂಟ್ ಕೈಲಾಷ್ ಪವರ್ ಪ್ರಾಜೆಕ್ಟ್ ಪ್ರೈವೇಟ್ ಲಿಮಿಟೆಡ್ ಇವರಿಗೆ ಉಡುಪಿ ಜಿಲ್ಲೆಯ ಕಾರ್ಕಳ ತಾಲ್ಲೂಕಿನ ಮುಚ್ಚಮೊಗರು ಹೊಳೆಗೆ (ಮಲ್ಲಿಬೆಟ್ಟು ಗ್ರಾಮ) ಅಡ್ಡಲಾಗಿ 6.00 ಮೆಗಾ ವ್ಯಾಟ್ ಸಾಮರ್ಥ್ಯದ ಕಿರುಜಲ ವಿದ್ಯುತ್ ಯೋಜನೆಯನ್ನು ಹಂಚಿಕೆ ಮಾಡಲಾಗಿತ್ತು. ತದ ನಂತರ ಮೇಲೆ ಓದಲಾದ ಕ್ರಮ ಸಂಖ್ಯೆ (2)ರ ಆದೇಶದಲ್ಲಿ ಯೋಜನೆಯ ಸಾಮರ್ಥ್ಯವನ್ನು 6.00 ಮೆಗಾ ವ್ಯಾಟ್‌ನಿಂದ 10.5 ಮೆಗಾ ವ್ಯಾಟ್‌ಗೆ ಹೆಚ್ಚಿಸಲಾಗಿತ್ತು.

ಮೇಲೆ ಓದಲಾದ ಕ್ರಮ ಸಂಖ್ಯೆ (3)ರ ಆದೇಶದಲ್ಲಿ ಸದರಿ ಯೋಜನೆಯ ಜಿಲ್ಲೆ ಮತ್ತು ತಾಲ್ಲೂಕಿನ ಹೆಸರನ್ನು ಉಡುಪಿ ಜಿಲ್ಲೆಯ ಕಾರ್ಕಳ ತಾಲ್ಲೂಕಿಗೆ ಬದಲಾಗಿ ದಕ್ಷಿಣ ಕನ್ನಡ ಜಿಲ್ಲೆಯ ಮಂಗಳೂರು ತಾಲ್ಲೂಕು ಎಂದು ಬದಲಾಯಿಸಿ ಆದೇಶಿಸಲಾಗಿತ್ತು.

ಮೇಲೆ ಓದಲಾದ ಕ್ರಮ ಸಂಖ್ಯೆ (4)ರ ಆದೇಶದಲ್ಲಿ ಮೆ॥ ಮೌಂಟ್ ಕೈಲಾಷ್ ಪವರ್ ಪ್ರಾಜೆಕ್ಟ್ ಪ್ರೈವೇಟ್ ಲಿಮಿಟೆಡ್ ಇವರಿಗೆ ಉಡುಪಿ ಜಿಲ್ಲೆಯ ಕಾರ್ಕಳ ತಾಲ್ಲೂಕಿನ ಮುಚ್ಚಮೊಗರು ಹೊಳೆಗೆ (ಮಲ್ಲಿಬೆಟ್ಟು ಗ್ರಾಮ) ಅಡ್ಡಲಾಗಿ ಹಂಚಿಕೆಯಾಗಿದ್ದ 10.5 ಮೆಗಾ ವ್ಯಾಟ್ ಸಾಮರ್ಥ್ಯದ ಕಿರು ಜಲ ವಿದ್ಯುತ್ ಯೋಜನೆಯ ಹಂಚಿಕೆ ಆದೇಶವನ್ನು ರದ್ದು ಪಡಿಸಲಾಗಿತ್ತು. ಮೇಲೆ ಓದಲಾದ ಕ್ರಮ ಸಂಖ್ಯೆ (5)ರ ಆದೇಶದಲ್ಲಿ ಈ ರದ್ದತಿ ಆದೇಶವನ್ನು ಹಿಂಪಡೆದು ಯೋಜನೆಯನ್ನು ಪೂರ್ವಸ್ಥಿತಿಗೆ ತರಲಾಗಿತ್ತು ಹಾಗೂ ಯೋಜನೆಯ ಅನುಷ್ಠಾನಕ್ಕಾಗಿ ಕಾಲಾವಕಾಶವನ್ನು ಆಗಸ್ಟ್ 2012ರವರೆಗೆ ವಿಸ್ತರಿಸಲಾಗಿತ್ತು.

ಭಾರತ ಸರ್ಕಾರದ ಕಾರ್ಪೋರೇಟ್ ಅಫೈರ್ಸ್ ಮಂತ್ರಾಲಯ, ರಿಜಿಸ್ಟ್ರಾರ್ ಆಫ್ ಕಂಪನೀಸ್, ಕರ್ನಾಟಕ ಇವರ CI No: U40101KA2002PTC031173 ದಿನಾಂಕ 31.7.2010ರಲ್ಲಿ ಮೆ॥ ಮೌಂಟ್ ಕೈಲಾಷ್ ಪವರ್ ಪ್ರಾಜೆಕ್ಟ್ ಪ್ರೈವೇಟ್ ಲಿಮಿಟೆಡ್ ಕಂಪನಿಯ ಹೆಸರನ್ನು ಮೆ : ಸೋಹಮ್ ಫಾಲ್ಗುಣಿ ರಿನ್ಯೂವೆಬಲ್ ಎನರ್ಜಿ ಪ್ರೈವೇಟ್ ಲಿಮಿಟೆಡ್ ಎಂದು ಬದಲಾಯಿಸಿ ಪ್ರಮಾಣ ಪತ್ರ ನೀಡಿರುವುದರಿಂದ, ಕಂಪನಿಯ ಹೆಸರು ಬದಲಾವಣೆ ಹಾಗೂ ಪ್ರತಿ ಮೆ.ವ್ಯಾ.ಗೆ ರೂ 3.00 ಲಕ್ಷಗಳ ನೆರವೇರಿಕೆ ಖಾತರಿ (Performance guarantee) ಮತ್ತು ಕಾಲಾವಕಾಶ ವಿಸ್ತರಣಾ ಶುಲ್ಕ ಪಾವತಿಸುವ ಷರತ್ತಿಗೊಳಪಟ್ಟು ಯೋಜನೆಯ ಅನುಷ್ಠಾನಕ್ಕೆ ಆಗಸ್ಟ್ 2014 ರವರೆಗೆ ಕಾಲಾವಕಾಶವನ್ನು ವಿಸ್ತರಿಸಲು ಮೇಲೆ ಓದಲಾದ ಕ್ರಮ ಸಂಖ್ಯೆ (6)ರ ಪತ್ರಗಳಲ್ಲಿ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ ವ್ಯವಸ್ಥಾಪಕ ನಿರ್ದೇಶಕರು ಶಿಫಾರಸ್ಸು ಮಾಡಿ ಪ್ರಸ್ತಾವನೆಯನ್ನು ಸರ್ಕಾರಕ್ಕೆ ಸಲ್ಲಿಸಿರುತ್ತಾರೆ.

ಸದರಿ ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ, ಈ ಕೆಳಗಿನಂತೆ ಆದೇಶಿಸಲಾಗಿದೆ:–

**ಸರ್ಕಾರಿ ಆದೇಶ ಸಂಖ್ಯೆ: ಇಎನ್ 254 ಎನ್‌ಸಿಇ 2012, ಬೆಂಗಳೂರು, ದಿನಾಂಕ: 10.12.2012.**

ಮೆ॥ ಮೌಂಟ್ ಕೈಲಾಷ್ ಪವರ್ ಪ್ರಾಜೆಕ್ಟ್ ಪ್ರೈವೇಟ್ ಲಿಮಿಟೆಡ್ ಕಂಪನಿಯ ಹೆಸರನ್ನು ಮೆ : ಸೋಹಮ್ ಫಾಲ್ಗುಣಿ ರಿನ್ಯೂವೆಬಲ್ ಎನರ್ಜಿ ಪ್ರೈವೇಟ್ ಲಿಮಿಟೆಡ್ ಎಂದು ಬದಲಾಯಿಸಿ ಆದೇಶಿಸಿದೆ ಹಾಗೂ ಸದರಿ ಕಂಪನಿಗೆ ದಕ್ಷಿಣ ಕನ್ನಡ ಜಿಲ್ಲೆಯ ಮಂಗಳೂರು ತಾಲ್ಲೂಕಿನ ಪುಚ್ಚಮೊಗರು ಹೊಳೆಗೆ (ಮಲ್ಲಿಬೆಟ್ಟು ಗ್ರಾಮ) ಅಡ್ಡಲಾಗಿ ಮಂಜೂರಾಗಿರುವ 10.5 ಮೆಗಾ ವ್ಯಾಟ್ ಸಾಮರ್ಥ್ಯದ ಕಿರು ಜಲ ವಿದ್ಯುತ್ ಯೋಜನೆಯ ಅನುಷ್ಠಾನಕ್ಕೆ ಅಂತಿಮವಾಗಿ ಮತ್ತು ಯಾವುದೇ ಕಾಲಾವಕಾಶ ವಿಸ್ತರಿಸುವುದಿಲ್ಲ ಹಾಗೂ ಈ ಕೆಳಕಂಡ ಷರತ್ತಿಗೊಳಪಟ್ಟು ಕಾಲಾವಕಾಶವನ್ನು ಸೆಪ್ಟೆಂಬರ್ 2012 ರಿಂದ ಆಗಸ್ಟ್ 2014 ರವರೆಗೆ ವಿಸ್ತರಿಸಲಾಗಿದೆ :–

1. ಅಭಿವೃದ್ಧಿದಾರರು ಮಾಹೆಯಾನ ಶೆಡ್ಯೂಲ್ ಆಫ್ ವರ್ಕ್‌ನ್ನು ಕೆ.ಆರ್.ಇ.ಡಿ.ಎಲ್.ಗೆ ನೀಡತಕ್ಕದ್ದು, ಕ್ರೆಡಲ್ ಪ್ರತಿ 3 ತಿಂಗಳಿಗೊಮ್ಮೆ ಯೋಜನಾ ಪ್ರಗತಿಯನ್ನು ಪರಿಶೀಲಿಸಿ ಸರ್ಕಾರಕ್ಕೆ ವರದಿ ನೀಡತಕ್ಕದ್ದು.
2. ಮೆಗಾ ವ್ಯಾಟ್ ಒಂದಕ್ಕೆ ರೂ 3.00 ಲಕ್ಷಗಳ ನೆರವೇರಿಕೆ ಖಾತರಿ (Performance guarantee) ಮತ್ತು ನಿಗದಿತ ಕಾಲಾವಕಾಶ ವಿಸ್ತರಣಾ ಶುಲ್ಕವನ್ನು ಪಾವತಿಸತಕ್ಕದ್ದು.
3. ಈ ಆದೇಶವನ್ನು ರದ್ದು ಪಡಿಸುವುದು/ಮಾರ್ಪಾಡು ಮಾಡುವ ಅಧಿಕಾರವನ್ನು ಸರ್ಕಾರವು ಹೊಂದಿರುತ್ತದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,
**ಕೌಸಲ್ಯಾ**
ಸರ್ಕಾರದ ಅಧೀನ ಕಾರ್ಯದರ್ಶಿ,
ಇಂಧನ ಇಲಾಖೆ.

**PR.2257**

## ಇಂಧನ ಸಚಿವಾಲಯ

**ವಿಷಯ:** ಮೆ:: ಎಸ್.ಸಿ.ಎಮ್. ಶುಗರ್ಸ್ ಕಂಪನಿಯ ಹೆಸರನ್ನು ಮೆ : ಎನ್.ಎಸ್.ಎಲ್. ಶುಗರ್ಸ್ ಲಿಮಿಟೆಡ್ ಎಂದು ಬದಲಾಯಿಸುವ ಬಗ್ಗೆ.

**ಓದಲಾಗಿದೆ:**
1) ಸರ್ಕಾರಿ ಪತ್ರ ಸಂಖ್ಯೆ: ಡಿಇ 3 ಎನ್‌ಸಿಇ 2000 ದಿನಾಂಕ: 26.2.2000
2) ಸರ್ಕಾರಿ ಆದೇಶ ಸಂಖ್ಯೆ: ಡಿಇ 3 ಎನ್‌ಸಿಇ 2000 ದಿನಾಂಕ: 11.12.2001.
3) ಸರ್ಕಾರಿ ಪತ್ರ ಸಂಖ್ಯೆ: ಡಿಇ 66 ಎನ್‌ಸಿಇ 2002 ದಿನಾಂಕ: 09.4.2002.
4) ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ, ವ್ಯವಸ್ಥಾಪಕ ನಿರ್ದೇಶಕರ ಪತ್ರ ಸಂಖ್ಯೆ: ಕೆಆರ್‌ಇಡಿಎಲ್/04/ಎನ್‌ಎಸ್‌ಎಲ್/2012–13/2797 ದಿನಾಂಕ: 02.11.2012.

**ಪ್ರಸ್ತಾವನೆ:–**

ಮೇಲೆ ಓದಲಾದ ಕ್ರಮ ಸಂಖ್ಯೆ (1) ರ ಪತ್ರದಲ್ಲಿ ಮೆ:: ಎಸ್.ಸಿ.ಎಮ್. ಶುಗರ್ಸ್ ಕಂಪನಿಗೆ ಮಂಡ್ಯ ಜಿಲ್ಲೆಯ ಮದ್ದೂರು ತಾಲ್ಲೂಕಿನ ಕೊಪ್ಪ ಗ್ರಾಮದಲ್ಲಿ 15 ಮೆ.ವ್ಯಾ (ಗ್ರಾಸ್) ಮತ್ತು 8.9 ಮೆ.ವ್ಯಾ. (ಎಕ್ಸ್‌ಪೋರ್ಟೆಬಲ್) ಸಾಮರ್ಥ್ಯದ ಸಹ ವಿದ್ಯುತ್ ಯೋಜನೆಯ ಘಟಕವನ್ನು ಸ್ಥಾಪಿಸಲು ನಿರಾಕ್ಷೇಪಣೆಯನ್ನು ನೀಡಲಾಗಿತ್ತು. ಸದರಿ ಸಾಮರ್ಥ್ಯವನ್ನು 26 ಮೆ.ವ್ಯಾ (ಗ್ರಾಸ್) ಮತ್ತು 13 ಮೆ.ವ್ಯಾ. ( Exportable during season) 24 ಮೆ.ವ್ಯಾ . ( Exportable during off season) ಗೆ ಮೇಲೆ ಓದಲಾದ ಕ್ರಮ ಸಂಖ್ಯೆ (2) ರ ಆದೇಶದಲ್ಲಿ ಹೆಚ್ಚಿಸಿ ಆದೇಶಿಸಲಾಗಿತ್ತು.

ಮೇಲೆ ಓದಲಾದ ಕ್ರಮ ಸಂಖ್ಯೆ (3) ರ ಪತ್ರದಲ್ಲಿ ಮೆ:: ಎಸ್.ಸಿ.ಎಮ್. ಶುಗರ್ಸ್ ಕಂಪನಿಗೆ ಮೇಲಿನಂತೆ ನೀಡಿರುವ ನಿರಾಕ್ಷೇಪಣೆಯ ಸಾಮರ್ಥ್ಯವನ್ನು 40 ಮೆ.ವ್ಯಾ. (ಗ್ರಾಸ್) ಮತ್ತು 20 ಮೆ.ವ್ಯಾ. ( Exportable during season) 36 ಮೆ.ವ್ಯಾ. ( Exportable during off season) ಸಾಮರ್ಥ್ಯಕ್ಕೆ ಹೆಚ್ಚಿಸಲಾಗಿತ್ತು.

ಭಾರತ ಸರ್ಕಾರದ ಕಾರ್ಪೋರೇಟ್ ವ್ಯವಹಾರಗಳ ಸಚಿವಾಲಯ, ರಿಜಿಸ್ಟ್ರಾರ್ ಆಫ್ ಕಂಪನೀಸ್, ಕರ್ನಾಟಕ ಇವರು CI No.: U15429KA1999PLCO26121 ದಿನಾಂಕ 10.7.2008ರಲ್ಲಿ ಮೆ:: ಎಸ್.ಸಿ.ಎಮ್. ಶುಗರ್ಸ್ ಕಂಪನಿಯ ಹೆಸರನ್ನು ಮೆ : ಎನ್.ಎಸ್.ಎಲ್. ಶುಗರ್ಸ್ ಲಿಮಿಟೆಡ್ ಎಂದು ಬದಲಾಯಿಸಿ ಪ್ರಮಾಣ ಪತ್ರ ನೀಡಿರುತ್ತಾರೆ ಈ ಹಿನ್ನೆಲೆಯಲ್ಲಿ ಮೇಲೆ ಕ್ರಮ ಸಂಖ್ಯೆ (4) ರಲ್ಲಿ ಓದಲಾದ ಪತ್ರದಲ್ಲಿ ವ್ಯವಸ್ಥಾಪಕ ನಿರ್ದೇಶಕರು, ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತ ರವರು ಮೆ:: ಎಸ್.ಸಿ.ಎಮ್. ಶುಗರ್ಸ್ ಕಂಪನಿಯ ಹೆಸರನ್ನು ಮೆ : ಎನ್.ಎಸ್.ಎಲ್. ಶುಗರ್ಸ್ ಲಿಮಿಟೆಡ್ ಎಂದು ಬದಲಾಯಿಸಿ ಸೂಕ್ತ ಆದೇಶ ಹೊರಡಿಸುವಂತೆ ಕೋರಿ ಪ್ರಸ್ತಾವನೆಯನ್ನು ಸಲ್ಲಿಸಿರುತ್ತಾರೆ.

ಸದರಿ ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ, ಈ ಕೆಳಗಿನಂತೆ ಆದೇಶಿಸಲಾಗಿದೆ:–

**ಸರ್ಕಾರಿ ಆದೇಶ ಸಂಖ್ಯೆ: ಇಎನ್ 344 ಎನ್‌ಸಿಇ 2012, ಬೆಂಗಳೂರು, ದಿನಾಂಕ: 10.12.2012.**

ಮೆ:: ಎಸ್.ಸಿ.ಎಮ್. ಶುಗರ್ಸ್ ಕಂಪನಿಯ ಹೆಸರನ್ನು ಮೆ:: ಎನ್.ಎಸ್.ಎಲ್. ಶುಗರ್ಸ್ ಲಿಮಿಟೆಡ್ ಎಂದು **ಬದಲಾಯಿಸಲು** ಅನುಮೋದನೆ ನೀಡಿದೆ. ಉಳಿದಂತೆ ಯಾವುದೇ ಬದಲಾವಣೆ ಇರುವುದಿಲ್ಲ.

ಈ ಆದೇಶವನ್ನು ರದ್ದು ಪಡಿಸುವುದು/ಮಾರ್ಪಾಡು ಮಾಡುವ ಅಧಿಕಾರವನ್ನು ಸರ್ಕಾರವು ಹೊಂದಿರುತ್ತದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,
**ಕೌಸಲ್ಯಾ**
ಸರ್ಕಾರದ ಅಧೀನ ಕಾರ್ಯದರ್ಶಿ,
ಇಂಧನ ಇಲಾಖೆ.

**PR.2259**

## ಒಳಾಡಳಿತ ಸಚಿವಾಲಯ

**ವಿಷಯ:** ನಕ್ಸಲ್ ಬಾಧಿತ ಪ್ರದೇಶಗಳ ಅಭಿವೃದ್ಧಿ ಕಾರ್ಯಕ್ರಮಗಳನ್ನು ಅನುಷ್ಠಾನಗೊಳಿಸಲು ರಾಜ್ಯ ಮಟ್ಟದ ಸಮಿತಿ ರಚಿಸುವ ಬಗ್ಗೆ

**ಓದಲಾಗಿದೆ:**
1. ಸರ್ಕಾರದ ಆದೇಶ ಸಂಖ್ಯೆ: ಹೆಚ್‌ಡಿ 283 ಎಸ್‌ಎಸ್‌ಟಿ 2012, ದಿನಾಂಕ:29/06/2012
2. ಸರ್ಕಾರದ ಆದೇಶ ಸಂಖ್ಯೆ: ಹೆಚ್‌ಡಿ 283 ಎಸ್‌ಎಸ್‌ಟಿ 2012, ದಿನಾಂಕ:17/07/2012
3. ಸರ್ಕಾರದ ಆದೇಶ ಸಂಖ್ಯೆ: ಎಫ್‌ಡಿ 43 ಬಿಆರ್‌ಎಸ್ 2012, ದಿನಾಂಕ:22/08/2012
4. ಸರ್ಕಾರದ ಆದೇಶ ಸಂಖ್ಯೆ: ಪಿಡಿ 77 ಪಿಎಂಎಂ 2012, ದಿನಾಂಕ:03/09/2012
5. ಸರ್ಕಾರದ ಅನಧಿಕೃತ ಟಿಪ್ಪಣಿ ಸಂಖ್ಯೆ: ಯೋಇ 77 ಯೋವಿವಿ 2012, ದಿನಾಂಕ:10/10/2012.

**ಪ್ರಸ್ತಾವನೆ:**

ಮೇಲೆ (1)ರಲ್ಲಿ ಓದಲಾದ ಸರ್ಕಾರಿ ಆದೇಶದಲ್ಲಿ ನಕ್ಸಲ್ ಬಾಧಿತ ಪ್ರದೇಶಗಳ ಸರ್ವಾಂಗೀಣ ಅಭಿವೃದ್ಧಿಗಾಗಿ ಆಯಾ ಜಿಲ್ಲೆಗಳ ಜಿಲ್ಲಾಧಿಕಾರಿಗಳ ನೇತೃತ್ವದಲ್ಲಿ ಉನ್ನತ ಅಧಿಕಾರಿಗಳ ಸಮಿತಿಯನ್ನು ರಚಿಸಲಾಗಿದೆ. ಮೇಲೆ (2) ಮತ್ತು (3)ರಲ್ಲಿ ಓದಲಾದ ಸರ್ಕಾರಿ ಆದೇಶಗಳಲ್ಲಿ 05 ಜಿಲ್ಲೆಗಳ 9 ನಕ್ಸಲ್ ಪೀಡಿತ ತಾಲ್ಲೂಕುಗಳ ಅಭಿವೃದ್ಧಿಗೆ ಒಟ್ಟು 45 ಕೋಟಿ ರೂಪಾಯಿಗಳ ಅನುದಾನವನ್ನು ಬಿಡುಗಡೆ ಮಾಡಲಾಗಿದೆ. ಮೇಲೆ ಓದಲಾದ (4)ರ ಸರ್ಕಾರಿ ಆದೇಶದಲ್ಲಿ ಒಟ್ಟು ರೂ.2250ಲಕ್ಷಗಳನ್ನು ಅಭಿವೃದ್ಧಿ ಕಾಮಾಗಾರಿಗಳನ್ನು ಕೈಗೆತ್ತಿಕೊಳ್ಳಲು ಬಿಡುಗಡೆ ಮಾಡಲಾಗಿದೆ. ನಕ್ಸಲ್ ಬಾಧಿತ ಪ್ರದೇಶಗಳ ಸರ್ವಾಂಗೀಣ ಅಭಿವೃದ್ಧಿಗಾಗಿ ನೀತಿ ಮತ್ತು ಕಾರ್ಯಕ್ರಮಗಳನ್ನು ರೂಪಿಸಲು ಹಾಗೂ ಅನುಷ್ಠಾನಗೊಳಿಸುವ ಕುರಿತು ಮಾರ್ಗದರ್ಶನ ನೀಡಲು ರಾಜ್ಯ ಮಟ್ಟದಲ್ಲಿ ಸರ್ಕಾರದ ಮುಖ್ಯ ಕಾರ್ಯದರ್ಶಿಗಳ ಅಧ್ಯಕ್ಷತೆಯಲ್ಲಿ ಸಂಬಂಧಪಟ್ಟ ಇಲಾಖೆಗಳ ಪ್ರಧಾನ ಕಾರ್ಯದರ್ಶಿ/ಕಾರ್ಯದರ್ಶಿಗಳನ್ನೊಳಗೊಂಡಂತೆ ಅಧಿಕಾರಯುಕ್ತ ಸಮಿತಿಯನ್ನು ರಚಿಸಲಾಗಿದೆ. ಆದರೆ ಇದರ ಬಗ್ಗೆ ಸೂಕ್ತ ಸರ್ಕಾರಿ ಆದೇಶವನ್ನು ಇದುವರೆವಿಗೂ ಹೊರಡಿಸಿರುವುದಿಲ್ಲ. ಈ ಸಮಿತಿಯು ಈಗಾಗಲೇ ಸಭೆ ಸೇರಿ ನಕ್ಸಲ್ ಪೀಡಿತ ಪ್ರದೇಶಗಳ ಅಭಿವೃದ್ಧಿ ಬಗ್ಗೆ ಜಿಲ್ಲಾಧಿಕಾರಿಗಳಿಗೆ ಸೂಕ್ತ ಮಾರ್ಗದರ್ಶನ ನೀಡಿದೆ. ಈ ಸಮಿತಿಯ ಶಿಫಾರಸ್ಸಿನ ಮೇರೆಗೆ ಮಾನ್ಯ ಮುಖ್ಯಮಂತ್ರಿಯವರು ದಿನಾಂಕ:15/06/2012ರಂದು ಸಭೆಯಲ್ಲಿ ಆದೇಶಿಸದಂತೆ ನಕ್ಸಲ್ ಪೀಡಿತ ಪ್ರದೇಶಗಳ ಅಭಿವೃದ್ಧಿಗಾಗಿ ಮೇಲೆ ತಿಳಿಸಿದಂತೆ ವಿಶೇಷ ಅನುದಾನವನ್ನು ಸರ್ಕಾರವು ಬಿಡುಗಡೆ ಮಾಡಿದೆ. ದಿನಾಂಕ:21/09/2012ರಂದು ನಡೆದ ಸಚಿವ ಸಂಪುಟದ ಸಭೆಯಲ್ಲಿಯೂ ಸಹ ನಕ್ಸಲ್ ಬಾಧಿತ ಪ್ರದೇಶಗಳ ಸರ್ವಾಂಗೀಣ ಅಭಿವೃದ್ಧಿ ಕುರಿತು ಕೈಗೊಂಡ ಕ್ರಮಗಳಿಗೆ ಹಾಗು ಅಧಿಕಾರಯುಕ್ತ ಸಮಿತಿ ರಚಿಸಿರುವ ಕ್ರಮಕ್ಕೆ ಘಟನೋತ್ತರ ಮಂಜೂರಾತಿ ನೀಡಲಾಗಿದೆ. ಮೇಲೆ (5)ರಲ್ಲಿ ಓದಲಾದ ಅನಧಿಕೃತ ಟಿಪ್ಪಣಿಯಲ್ಲಿ ಸರ್ಕಾರದ ಅಧೀನ ಕಾರ್ಯದರ್ಶಿ 1 & 2, ಯೋಜನೆ, ಕಾರ್ಯಕ್ರಮ ಸಂಯೋಜನೆ ಮತ್ತು ಸಾಂಖ್ಯಿಕ ಇಲಾಖೆ ಅವರು ಸಮಿತಿ ರಚನೆ ಬಗ್ಗೆ ಹಾಗೂ ಸಚಿವ ಸಂಪುಟದ ತೀರ್ಮಾನದ ಬಗ್ಗೆ ಕ್ರಮ ಕೈಗೊಳ್ಳಲು ಕೋರಿರುತ್ತಾರೆ. ಸರ್ಕಾರವು ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿದೆ. ಅದುದರಿಂದ ಈ ಆದೇಶ.

**ಸರ್ಕಾರಿ ಆದೇಶ ಸಂಖ್ಯೆ:ಹೆಚ್‌ಡಿ 283 ಎಸ್‌ಎಸ್‌ಟಿ 2012 ಬೆಂಗಳೂರು, ದಿನಾಂಕ:20/11/2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶಗಳ ಹಿನ್ನೆಲೆಯಲ್ಲಿ ನಕ್ಸಲ್ ಬಾಧಿತ ಪ್ರದೇಶಗಳ ಸರ್ವಾಂಗೀಣ ಅಭಿವೃದ್ಧಿಗಾಗಿ ನೀತಿ ಮತ್ತು ಕಾರ್ಯಕ್ರಮಗಳನ್ನು ರೂಪಿಸಲು ಹಾಗೂ ಅನುಷ್ಠಾನಗೊಳಿಸುವ ಕುರಿತು ಮಾರ್ಗದರ್ಶನ ನೀಡಲು ಸರ್ಕಾರದ ಮುಖ್ಯ ಕಾರ್ಯದರ್ಶಿಗಳ ಅಧ್ಯಕ್ಷತೆಯಲ್ಲಿ ಈ ಕೆಳಕಂಡ ಇಲಾಖೆಗಳ ಪ್ರಧಾನ ಕಾರ್ಯದರ್ಶಿಗಳು/ಕಾರ್ಯದರ್ಶಿಗಳನ್ನೊಳಗೊಂಡ ರಾಜ್ಯ ಮಟ್ಟದ ಅಧಿಕಾರಯುಕ್ತ ಸಮಿತಿಯನ್ನು ರಚಿಸಿದೆ.

| | | |
|---|---|---|
| 1 | ಸರ್ಕಾರದ ಮುಖ್ಯ ಕಾರ್ಯದರ್ಶಿ | ಅಧ್ಯಕ್ಷರು |
| 2 | ಸರ್ಕಾರದ ಅಪರ ಮುಖ್ಯ ಕಾರ್ಯದರ್ಶಿ ಹಾಗೂ ಅಭಿವೃದ್ಧಿ ಆಯುಕ್ತರು | ಉಪಾಧ್ಯಕ್ಷರು |
| 3 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಒಳಾಡಳಿತ ಇಲಾಖೆ | ಸದಸ್ಯ ಕಾರ್ಯದರ್ಶಿ |
| 4 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಯೋಜನಾ ಇಲಾಖೆ | ಸದಸ್ಯರು |
| 5 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಆರ್ಥಿಕ ಇಲಾಖೆ | ಸದಸ್ಯರು |
| 6 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆ | ಸದಸ್ಯರು |
| 7 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ | ಸದಸ್ಯರು |
| 8 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಶಿಕ್ಷಣ ಇಲಾಖೆ | ಸದಸ್ಯರು |
| 9 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಕಂದಾಯ ಇಲಾಖೆ | ಸದಸ್ಯರು |
| 10 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಇಲಾಖೆ | ಸದಸ್ಯರು |

| | | |
|---|---|---|
| 11 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಕಾರ್ಮಿಕ ಇಲಾಖೆ | ಸದಸ್ಯರು |
| 12 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ವಸತಿ ಇಲಾಖೆ | ಸದಸ್ಯರು |
| 13 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಅರಣ್ಯ, ಪರಿಸರ ಮತ್ತು ಜೀವಿಶಾಸ್ತ್ರ ಇಲಾಖೆ | ಸದಸ್ಯರು |
| 14 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಸಾರಿಗೆ ಇಲಾಖೆ | ಸದಸ್ಯರು |
| 15 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಸಮಾಜ ಕಲ್ಯಾಣ ಇಲಾಖೆ | ಸದಸ್ಯರು |
| 16 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಕೃಷಿ ಇಲಾಖೆ | ಸದಸ್ಯರು |
| 17 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಆಹಾರ ಮತ್ತು ನಾಗರೀಕ ಸರಬರಾಜು ಇಲಾಖೆ | ಸದಸ್ಯರು |
| 18 | ಸರ್ಕಾರದ ಪ್ರಧಾನ ಕಾರ್ಯದರ್ಶಿ, ಲೋಕೋಪಯೋಗಿ ಇಲಾಖೆ | ಸದಸ್ಯರು |
| 19 | ಜಿಲ್ಲಾಧಿಕಾರಿಗಳು, ದಕ್ಷಿಣ ಕನ್ನಡ, ಉಡುಪಿ, ಚಿಕ್ಕಮಗಳೂರು, ಶಿವಮೊಗ್ಗ, ತುಮಕೂರು ಜಿಲ್ಲೆಗಳು | ಸದಸ್ಯರು |
| 20 | ಆರಕ್ಷಕ ಮಹಾ ನಿರೀಕ್ಷಕರು, ರಾಜ್ಯ ಗುಪ್ತ ವಾರ್ತೆ | ಸದಸ್ಯರು |
| 21 | ಆರಕ್ಷಕ ಮಹಾ ನಿರೀಕ್ಷಕರು, ನಕ್ಸಲ್ ನಿಗ್ರಹ ದಳ | ಸದಸ್ಯರು |
| 22 | ಮುಖ್ಯ ಕಾರ್ಯ ನಿರ್ವಹಣಾಧಿಕಾರಿಗಳು, ದಕ್ಷಿಣ ಕನ್ನಡ, ಉಡುಪಿ, ಚಿಕ್ಕಮಗಳೂರು, ಶಿವಮೊಗ್ಗ, ತುಮಕೂರು ಜಿಲ್ಲೆಗಳು | ಸದಸ್ಯರು |

2) ರಾಜ್ಯಮಟ್ಟದ ಸಮಿತಿಯು ನಕ್ಸಲ್ ಬಾಧಿತ ಪ್ರದೇಶಗಳ ಅಭಿವೃದ್ಧಿ ಕಾರ್ಯಗಳ ನಿರಂತರ ಮೇಲ್ವಿಚಾರಣೆಯನ್ನು ಮಾಡುವುದು.

3) ರಾಜ್ಯ ಗುಪ್ತವಾರ್ತೆಯವರು ನೀಡುವ ವರದಿಯನ್ನು ಅಭ್ಯಸಿಸಿ ನಕ್ಸಲ್ ಬಾಧಿತ ಪ್ರದೇಶಗಳನ್ನು ಸೇರಿಸುವ ಅಥವಾ ತೆಗೆದು ಹಾಕುವ ನಿರ್ಣಯವನ್ನು ತೆಗೆದುಕೊಳ್ಳುವುದು.

4) ಜಿಲ್ಲಾಧಿಕಾರಿಗಳ ನೇತೃತ್ವದಲ್ಲಿ ರಚಿಸಲಾಗಿರುವ ಸಮಿತಿಗೆ ಸೂಕ್ತ ಮಾರ್ಗದರ್ಶನ ನೀಡುವುದು.

5) ಅಭಿವೃದ್ಧಿ ಕಾರ್ಯಗಳನ್ನು ಜಾರಿಗೊಳಿಸುವಲ್ಲಿ ಉಂಟಾಗಬಹುದಾದ ಯಾವುದೇ ರೀತಿಯ ಕೊರತೆಗಳನ್ನು ನೀಗಿಸಲು ಕಾರ್ಯಕ್ರಮಗಳನ್ನು/ ಮಾರ್ಗೋಪಾಯಗಳನ್ನು ಸೂಚಿಸುವುದು.

6) ರಾಜ್ಯ ಮಟ್ಟದ ಸಮಿತಿಯು 4 ತಿಂಗಳಿಗೊಮ್ಮೆ ಸಭೆ ಸೇರಿ ಪರಿಶೀಲನೆ ನಡೆಸುವುದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ.

**ಪ್ರಕಾಶ ವೈ.ಕೆ.**

ಸರ್ಕಾರದ ಅಧೀನ ಕಾರ್ಯದರ್ಶಿ,

**PR.2207** ಒಳಾಡಳಿತ ಇಲಾಖೆ,(ಕಾನೂನು ಮತ್ತು ಸುವ್ಯವಸ್ಥೆ)

## ಒಳಾಡಳಿತ ಸಚಿವಾಲಯ

**ವಿಷಯ:** ಭಾರತೀಯ ನಾಗರೀಕರಿಗೆ ಪೊಲೀಸ್ ಕ್ಲಿಯರೆನ್ಸ್ ಸರ್ಟಿಫಿಕೇಟ್ ನೀಡಲು ಶುಲ್ಕ ನಿಗದಿಪಡಿಸುವ ಬಗ್ಗೆ.

**ಉಲ್ಲೇಖ:** 1. ಸರ್ಕಾರದ ಆದೇಶ ಸಂಖ್ಯೆ:ಹೆಚ್‌ಡಿ 230 ಪಿಎಂಎಸ್ 2002, ದಿ31/03/2004

2. ಪೊಲೀಸ್ ಆಯುಕ್ತರು, ಬೆಂಗಳೂರು ನಗರ, ಬೆಂಗಳೂರು ಇವರ ಪತ್ರ ಸಂಖ್ಯೆ:ಎಸ್‌ಬಿ/ಬಿಸಿ/ಆಡಳಿತ/51/2012, ದಿನಾಂಕ:08/03/2012.

**ಪ್ರಸ್ತಾವನೆ:–**

ಉಲ್ಲೇಖ(1)ರಲ್ಲಿ ಓದಲಾದ ಸರ್ಕಾರಿ ಆದೇಶದಲ್ಲಿ ವಿದೇಶಿಯರಿಗೆ ಪೊಲೀಸ್ ಕ್ಲಿಯರೆನ್ಸ್ ಸರ್ಟಿಫಿಕೇಟ್ ನೀಡುವ ಸಂಬಂಧ ರೂ.200/– (ರೂಪಾಯಿ ಎರಡು ನೂರು ಮಾತ್ರ) ಪ್ರತಿ ಅಭ್ಯರ್ಥಿಯಿಂದ ಪಡೆಯಲು ಪೊಲೀಸ್ ಆಯುಕ್ತರು, ಬೆಂಗಳೂರು, ಮೈಸೂರು ಮತ್ತು ಹುಬ್ಬಳ್ಳಿ–ಧಾರವಾಡ ಹಾಗೂ ಇನ್ನುಳಿದ ಜಿಲ್ಲೆಗಳ ಪೊಲೀಸ್ ಅಧೀಕ್ಷಕರುಗಳಿಗೆ ಅಧಿಕಾರ ನೀಡಲಾಗಿದೆ.

ಉಲ್ಲೇಖ(2)ರಲ್ಲಿ ಓದಲಾದ ಪತ್ರದಲ್ಲಿ ಪೊಲೀಸ್ ಆಯುಕ್ತರು, ಬೆಂಗಳೂರು ಅವರು ವಿದೇಶಿಯವರಿಗೆ ಶುಲ್ಕವನ್ನು ನಿಗದಿಪಡಿಸಿರುವ ಮಾದರಿಯಲ್ಲಿ ಭಾರತೀಯ ನಾಗರೀಕರಿಗೂ ಪೊಲೀಸ್ ಕ್ಲಿಯರೆನ್ಸ್ ಸರ್ಟಿಫಿಕೇಟ್ ಪಡೆಯಲು ರೂ.200/– (ರೂಪಾಯಿ ಎರಡು ನೂರು ಮಾತ್ರ) ನಿಗಧಿಗೊಳಿಸುವಂತೆ ಸರ್ಕಾರವನ್ನು ಕೋರಿರುತ್ತಾರೆ. ಅದರಂತೆ ಈ ಆದೇಶ.

**ಸರ್ಕಾರದ ಆದೇಶ ಸಂಖ್ಯೆ: ಹೆಚ್‌ಡಿ 130 ಎಸ್‌ಎಸ್‌ಟಿ 2011, ಬೆಂಗಳೂರು ದಿನಾಂಕ: 12/09/2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಅಂಶದ ಹಿನ್ನೆಲೆಯಲ್ಲಿ ವಿದೇಶಿಯರು ಪೊಲೀಸ್ ಕ್ಲಿಯರೆನ್ಸ್ ಸರ್ಟಿಫಿಕೇಟ್ ಪಡೆಯಲು ನಿಗದಿಪಡಿಸಿರುವ ಶುಲ್ಕದ ಮಾದರಿಯಲ್ಲೇ ಭಾರತೀಯ ನಾಗರೀಕರು ಪೊಲೀಸ್ ಕ್ಲಿಯರೆನ್ಸ್ ಸರ್ಟಿಫಿಕೇಟ್ ಪಡೆಯಲು ರೂ.200/– (ರೂಪಾಯಿ ಎರಡು ನೂರು ಮಾತ್ರ) ಪ್ರತಿ ಅಭ್ಯರ್ಥಿಯಿಂದ ಪಡೆಯಲು ಪೊಲೀಸ್ ಆಯುಕ್ತರು, ಬೆಂಗಳೂರು, ಮೈಸೂರು ಮತ್ತು ಹುಬ್ಬಳ್ಳಿ–ಧಾರವಾಡ, ಮಂಗಳೂರು ಹಾಗೂ ಇನ್ನುಳಿದ ಜಿಲ್ಲೆಗಳ ಪೊಲೀಸ್ ಅಧೀಕ್ಷಕರುಗಳಿಗೆ ಅಧಿಕಾರ ನೀಡಿ ಶುಲ್ಕವನ್ನು ನಿಗಧಿಪಡಿಸಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆ ಟಿಪ್ಪಣಿ ಸಂಖ್ಯೆ:ಎಫ್‌ಡಿ/299/ವೆಚ್ಚ–11/2012 ದಿನಾಂಕ 31/08/2012ರಲ್ಲಿ ನೀಡಿರುವ ಸಹಮತಿ ಮೇರೆಗೆ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ.

**ಪ್ರಕಾಶ ವೈ.ಕೆ.**

ಸರ್ಕಾರದ ಅಧೀನ ಕಾರ್ಯದರ್ಶಿ,

**PR.2183** ಒಳಾಡಳಿತ ಇಲಾಖೆ,(ಕಾನೂನು ಮತ್ತು ಸುವ್ಯವಸ್ಥೆ)

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** 2012–13ನೇ ಸಾಲಿನ ಸಣ್ಣ ನೀರಾವರಿ ಸವಿವರ ಅಂದಾಜುಗಳು ಅನುಬಂಧ–"ಇ" ನಲ್ಲಿ ಸೇರಿರುವ ಕಾಮಗಾರಿಗಳಿಗೆ ಆಡಳಿತಾತ್ಮಕ ಅನುಮೋದನೆ ನೀಡಲು ಅಂದಾಜು ಮೊತ್ತದ ಶೇ.1/3 ಭಾಗದ ಕೊರತೆಯಿರುವ ಮೊತ್ತವನ್ನು ಮರುಹೊಂದಾಣಿಕೆ ಮೂಲಕ ಒದಗಿಸಿಕೊಳ್ಳುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ: ಮುಇಂ/ ಸನೀ(ಉ)ವ/ ಬಿಜೆಪಿ/ ಪಿಬಿ–4/ 2012–13/6194, ದಿನಾಂಕ 17.11.2012.

**ಪ್ರಸ್ತಾವನೆ:**

2012–13ನೇ ಸಾಲಿನ ಆಯವ್ಯಯದ "ಅನುಬಂಧ–ಇ" ನಲ್ಲಿ ಲೆಕ್ಕ ಶೀರ್ಷಿಕೆ **"4702–00–796–0–00–423 ಗಿರಿಜನ ಉಪಯೋಜನೆ"** ಅಡಿಯಲ್ಲಿ ಅಂದಾಜು ಮೊತ್ತದ ಶೇ.1/3ರಷ್ಟು ಅನುದಾನದೊಂದಿಗೆ ಸೇರಿರುವ ಬಿಜಾಪುರ ಸಣ್ಣ ನೀರಾವರಿ ವಿಭಾಗದ ವ್ಯಾಪ್ತಿಯ ಕಾಮಗಾರಿಗಳ ಅಂದಾಜುಗಳನ್ನು ವಾಸ್ತವಾಂಶಗಳಂತೆ ತಯಾರಿಸಲಾಗಿದ್ದು, ಕೆಲವೊಂದು ಕಾಮಗಾರಿಗಳ ಅಂದಾಜು ಮೊತ್ತ ಹೆಚ್ಚಾಗಿದೆ. ಅದೇ ರೀತಿ ಕೆಲವೊಂದು ಕಾಮಗಾರಿಗಳಲ್ಲಿ ಕಡಿಮೆಯಾಗಿವೆ. ಅಂದಾಜು ಮೊತ್ತ ಹೆಚ್ಚಾಗಿರುವ ಕಾಮಗಾರಿಗಳಿಗೆ ಆಡಳಿತಾತ್ಮಕ ಅನುಮೋದನೆ ನೀಡಲು ಆಯವ್ಯಯದಲ್ಲಿ ನಿಗದಿಪಡಿಸಿರುವ ಅನುದಾನ, ವಾಸ್ತವಿಕ ಅಂದಾಜು ಮೊತ್ತದ ಶೇ.1/3ರ ಮೊತ್ತಕ್ಕಿಂತ ಕಡಿಮೆಯಾಗುತ್ತದೆ. ಅದೇ ರೀತಿ ಕೆಲವೊಂದು ಕಾಮಗಾರಿಗಳ ವಾಸ್ತವಿಕ ಅಂದಾಜು ಮೊತ್ತವು ಕಡಿಮೆಯಾಗುತ್ತಿರುವುದರಿಂದ ಕಾಮಗಾರಿಗೆ ನಿಗದಿಪಡಿಸಿರುವ ಅನುದಾನ ಅಂದಾಜು ಮೊತ್ತದ ಶೇ.1/3ರ ಮೊತ್ತಕ್ಕಿಂತ ಹೆಚ್ಚಾಗುತ್ತಿದೆ. ಈ ರೀತಿ ಹೆಚ್ಚಾಗುತ್ತಿರುವ ಅನುದಾನವನ್ನು ಕಡಿಮೆ ಅನುದಾನವಿರುವ ಕಾಮಗಾರಿಗಳಿಗೆ ಮರುಹೊಂದಾಣಿಕೆ ಮಾಡಿಕೊಳ್ಳಲು ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರರವರು ಸರ್ಕಾರದ ಅನುಮೋದನೆಯನ್ನು ಕೋರಿರುತ್ತಾರೆ. ಪ್ರಸ್ತಾಪಿಸಿರುವ ಕಾಮಗಾರಿಗಳ ವಿವರ ಕೆಳಕಂಡಂತಿದೆ:

1ಅ) ಗಿರಿಜನ ಉಪಯೋಜನೆ ಶೀರ್ಷಿಕೆಯಡಿ ಅನುಮೋದನೆಯಾಗಿರುವ ಕಾಮಗಾರಿಗಳ ಅಂದಾಜಿನ ಶೇ.1/3ಕ್ಕೆ ಕೊರತೆಯಿರುವ ಕಾಮಗಾರಿಗಳ ವಿವರ ಕೆಳಕಂಡಂತಿದೆ:

(ಲಕ್ಷ ರೂ.ಗಳಲ್ಲಿ)

| ಕ್ರ. ಸಂ. | ಕಾಮಗಾರಿಯ ವಿವರ | ಲೆಕ್ಕ ಶೀರ್ಷಿಕೆ | ಆಯವ್ಯಯ ದಲ್ಲಿರುವಂತೆ ಅಂದಾಜು ಮೊತ್ತ /ವಾಸ್ತವಿಕ ಅಂದಾಜು ಮೊತ್ತ | ಆಯವ್ಯಯ ದಲ್ಲಿ ಒದಗಿಸಿರುವ ಅನುದಾನ | ವಾಸ್ತವಿಕ ಅಂದಾಜಿನ ಶೇ.1/3ಕ್ಕೆ ಕೊರತೆಯಿರುವ ಮೊತ್ತ |
|---|---|---|---|---|---|
| 1 | ಮುಧೋಳ ತಾಲೂಕಿನ ಬಂಟನೂರ ಗ್ರಾಮದ ಶ್ರೀ ರಂಗಪ್ಪ. ಬಾಲಪ್ಪ. ನಾಯಕ ಹಾಗೂ ಇತರರ ಜಮಿನುಗಳಿಗೆ ಏತ ನೀರಾವರಿ ಸೌಲಭ್ಯ ಒದಗಿಸುವದು (ಸ.ನಂ 1/10,65/2,12/5,65/7,11/5 ಹಾಗೂ ಇತರೆ). (ಪು.ಸಂ:329 ಕ್ರ.ಸಂ.110) | 4702–00–796–0–00–423 ಗಿರಿಜನ ಉಪಯೋಜನೆ | 35.00<br>40.00 | 11.67 | 1.67 |
| 2 | ಜಮಖಂಡಿ ತಾಲೂಕಿನ ನಾವಲಗಿ ಗ್ರಾಮದ ಸ.ನಂ., 270/3,4,273/3,4,268/7 ಮಲ್ಲಪ್ಪ. ಬಸಪ್ಪ. ಜಕನೂರ ಹಾಗೂ ಇತರರ ಹೊಲಗಳಿಗೆ ಕೊಳವೆ ಭಾವಿ ಮೂಲಕ ನೀರಾವರಿ ಸೌಲಭ್ಯ ಒದಗಿಸುವದು (ಪು.ಸಂ:329 ಕ್ರ.ಸಂ.111) | | 25.00<br>33.50 | 8.33 | 2.83 |
| | | | | **ಒಟ್ಟು:** | **4.50** |

1ಆ) 4702–00–101–5–01–139 ಅಣೆಕಟ್ಟು ಮತ್ತು ಪಿಕಪ್ –ಪ್ರಧಾನ ಕಾಮಗಾರಿಗಳು ಶೀರ್ಷಿಕೆಯಡಿ ಅನುಮೋದನೆಯಾಗಿರುವ ಕಾಮಗಾರಿಗಳಲ್ಲಿ ಅನುದಾನ ಉಳಿತಾಯವಾಗುತ್ತಿರುವ ಕಾಮಗಾಯ ವಿವರ:

(ಲಕ್ಷ ರೂ.ಗಳಲ್ಲಿ)

| ಕ್ರ ಸಂ | ಕಾಮಗಾರಿಯ ವಿವರ | ಲೆಕ್ಕ ಶೀರ್ಷಿಕೆ | ಆಯವ್ಯಯ ದಲ್ಲಿ ಒದಗಿಸಿರುವ ಅನುದಾನ | ಉಳಿತಾಯ ವಾಗುವ ಅನುದಾನದ ಮೊತ್ತ |
|---|---|---|---|---|
| 1 | ಮುಧೋಳ ತಾಲೂಕಿನ ಬುದ್ನಿ ಕೆ.ಡಿ ಗ್ರಾಮದ ಲಕ್ಷ್ಮನ.ಹನಮಂತ.ಗಡ್ಡಿ ಹಾಗೂ ಇತರರ ಹೊಲಗಳಿಗೆ ಏ.ನೀಯೋ ನೀರಾವರಿ ಸೌಲಭ್ಯ ಒದಗಿಸುವದು (ಸ.ನಂ 70,75,76 ಹಾಗೂ ಇತರೆ –ಮು.ಸಂ:328 ಕ್ರ.ಸಂ.108) | 4702–00–796–0–00–423 ಗಿರಿಜನ ಉಪಯೋಜನೆ | 10.00 | 4.00 |
| 2 | ಮುಧೋಳ ತಾಲೂಕಿನ ಮಲ್ಲಾಪೂರ ಗ್ರಾಮದ ಹತ್ತಿರ ಶ್ರೀಮತಿ ಲಕ್ಷ್ಮವ್ವ. ಹನಮಂತ ಕುಡಚಿ ಹಾಗೂ ಇತರರ ಹೊಲಗಳಿಗೆ ಕೋಳವೆ ಬಾವಿ ಮೂಲಕ ನೀರಾವರಿ ಸೌಲಭ್ಯ ಒದಗಿಸುವದು (ಸ.ನಂ 38/3ಬ , 38/2 ಹಾಗೂ ಇತರೆ –ಮು.ಸಂ:328 ಕ್ರ.ಸಂ.106) | 4702–00–796–0–00–423 ಗಿರಿಜನ ಉಪಯೋಜನೆ | 4.00 | 4.00 |
| | | | **ಒಟ್ಟು** | **8.00** |

ಪ್ರಸ್ತಾವನೆಯನ್ನು ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಸನೀಇ 03 ಮಸಾವಿ (ತಾಂತ್ರಿಕ) 2013 ಬೆಂಗಳೂರು, ದಿನಾಂಕ: 16ನೇ ಜನವರಿ 2013.**

ಮುಖ್ಯ ಇಂಜಿನಿಯರ್‌ರವರ ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ 2012–13ನೇ ಸಾಲಿನ ಆಯವ್ಯಯದ "ಅಪೆಂಡಿಕ್ಸ್–ಇ" ನಲ್ಲಿ ಲೆಕ್ಕ ಶೀರ್ಷಿಕೆ **"4702–00–796–0–00–423 ಗಿರಿಜನ ಉಪಯೋಜನೆ"** ಅಡಿಯಲ್ಲಿ ಸೇರಿರುವ ಪ್ರಸ್ತಾವನೆಯ ಕಂಡಿಕೆ 1(ಅ)ರಲ್ಲಿ ತಿಳಿಸಿರುವ ಎರೆಡು ಕಾಮಗಾರಿಗಳ ಅಂದಾಜು ಪಟ್ಟಿಗೆ ಆಡಳಿತಾತ್ಮಕ ಅನುಮೋದನೆ ನೀಡಲು ಅಂದಾಜಿನ ಮೊತ್ತದ ಶೇ.1/3ಕ್ಕಿಂತ ಕಡಿಮೆ ಇರುವ ಒಟ್ಟು 4.50ಲಕ್ಷ ರೂ.ಗಳ (ನಾಲ್ಕು ಲಕ್ಷ ಐವತ್ತು ಸಾವಿರ ರೂ.ಗಳು ಮಾತ್ರ) ಮೊತ್ತವನ್ನು ಪ್ರಸ್ತಾವನೆಯ ಕಂಡಿಕೆ 1(ಆ)ರಲ್ಲಿ ತಿಳಿಸಿರುವ ಎರೆಡು ಕಾಮಗಾರಿಗಳ ಆಯವ್ಯಯದಲ್ಲಿ ಒದಗಿಸಿರುವ ಅನುದಾನದಲ್ಲಿ ಉಳಿತಾಯವಾಗುವ ಒಟ್ಟು 8.00ಲಕ್ಷ ರೂ.ಗಳ (ಎಂಟು ಲಕ್ಷ ರೂ.ಗಳು ಮಾತ್ರ) ಅನುದಾನದಿಂದ ಮರು ಹೊಂದಾಣಿಕೆ ಮಾಡಿಕೊಂಡು ಭರಿಸಲು ಸರ್ಕಾರವು ಅನುಮೋದನೆ ನೀಡಿದೆ.

2) ಈ ಆದೇಶವನ್ನು ಸರ್ಕಾರದ ಆದೇಶ ಸಂಖ್ಯೆ:ಎಫ್‌ಡಿ 11 ಟಿಎಫ್‌ಪಿ 2007, ದಿನಾಂಕ 27/11/07ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ಪ್ರತ್ಯಾಯೋಜಿಸಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ರುದ್ರಮೂರ್ತಿ**

ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ,

ಜಲ ಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ).

**PR.169**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಯಾದಗೀರ್ ಜಿಲ್ಲೆ ಮತ್ತು ತಾಲ್ಲೂಕಿನ ದೊಡ್ಡಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011–12/4885, ದಿನಾಂಕ 21/09/2012.

**ಪ್ರಸ್ತಾವನೆ:**

ಯಾದಗೀರ್ ಜಿಲ್ಲೆ ಮತ್ತು ತಾಲ್ಲೂಕಿನ ದೊಡ್ಡಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಮುಂಡರಗಿ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಮ ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 16/04/1992.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 19/04/1994.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನ ಕಾಯ್ದೆ ಕಲಂ 11ರಡಿ ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಯಾದಗೀರ್ ಸಿವಿಲ್ ಜಡ್ಜ್(ಹಿರಿಯ ವಿಭಾಗ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣ ಸಂಖ್ಯೆ:24/1999ನ್ನು ದಾಖಲಿಸಿದ್ದು, ನ್ಯಾಯಾಲಯವು ಪ್ರತಿ ಎಕರೆ ಜಮೀನಿಗೆ ರೂ.15,000/–ಗಳನ್ನು ನಿಗದಿಪಡಿಸಿ ಆದೇಶಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು

ಕಂದಾಯ ಇಲಾಖೆಯ ಕಾನೂನು ಕೋಶವು ಪತ್ರ ಸಂಖ್ಯೆ:ಆರ್‌ಡಿ 571 ಎಲ್‌ಸಿಜಿ 2008, ದಿನಾಂಕ 02/09/2009ರಲ್ಲಿ ಅಭಿಪ್ರಾಯ ನೀಡಿದೆ. ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ. ಸಂ. | ಎಲ್‌ಎಸಿ | ಮುಂಡರಗಿ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|
| 1 | 24/1999 | 52/2 | 4–36 | 244247 |
| | | 47 | 19–06 | 1005879 |
| | | 48/2 | 0–24 | 31516 |
| | | | **ಒಟ್ಟು** | **1281642** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 147 ಭೂಸ್ವಾಪ್ರ 2011, ಬೆಂಗಳೂರು, ದಿನಾಂಕ 21ನೇ ಡಿಸೆಂಬರ್ 2012.**

ಯಾದಗೀರ್ ಜಿಲ್ಲೆ ಮತ್ತು ತಾಲ್ಲೂಕಿನ ದೊಡ್ಡಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಮುಂಡರಗಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.12,81,642–00ಗಳನ್ನು (ಹನ್ನೆರಡು ಲಕ್ಷದ ಎಂಭತ್ತೊಂದು ಸಾವಿರದ ಆರುನೂರ ನಲವತ್ತೆರಡು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ರೂ.12,81,642/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR.178**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಕಲಮೂಡ ಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/ 2012–13/6142 ದಿನಾಂಕ 17/11/2012.

**ಪ್ರಸ್ತಾವನೆ:**

ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಕಲಮೂಡ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಕಲಮೂಡ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 29/01/2004.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 03/01/2006.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಪಡೆದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಸಿವಿಲ್ ನ್ಯಾಯಾಲಯ(ಹಿರಿಯ ಶ್ರೇಣಿ) ಗುಲ್ಬರ್ಗಾ ಇಲ್ಲಿ ಎಲ್.ಎ.ಸಿ. ಪ್ರಕರಣ ಸಂಖ್ಯೆ: 193/2006ನ್ನು ದಾಖಲಿಸಿದ್ದು, ನ್ಯಾಯಾಲಯವು ದಿನಾಂಕ 18/01/2007ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ರೂ.66,300/–ಗಳನ್ನು ನಿಗದಿಪಡಿಸಿ ಆದೇಶಿಸಿದೆ. ಸಿವಿಲ್ ನ್ಯಾಯಾಲಯದ ತೀರ್ಪಿಗೆ ತೃಪ್ತರಾಗದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಗುಲ್ಬರ್ಗಾ ಜಿಲ್ಲಾ ನ್ಯಾಯಾಲಯದಲ್ಲಿ ಮೇಲ್ಮನವಿ ಎಲ್.ಎ.ಸಿ.ಎ.ಪ್ರಕರಣ ಸಂಖ್ಯೆ: 35/2011ನ್ನು ದಾಖಲಿಸಿದ್ದು, ಜಿಲ್ಲಾ ನ್ಯಾಯಾಲಯವು ದಿನಾಂಕ

11/11/2011ರಂದು ನೀಡಿದ ಆದೇಶದಲ್ಲಿ ರೂ.1,38,660/–ಗಳಿಗೆ ಹೆಚ್ಚಿಸಿ ಆದೇಶಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಅಧಿಕಾರಿ–3(ಎಲ್.ಎ.ಸಿ) ಇವರ ಪತ್ರ ಸಂಖ್ಯೆ: ಆರ್‌ಡಿ 23 ಎಲ್‌ಸಿಜಿ 2012, ದಿನಾಂಕ 20/06/2012ರಂದು ಅಭಿಪ್ರಾಯ ನೀಡಿದೆ. ನ್ಯಾಯಾಲಯವು ಹೆಚ್ಚಿನ ಪರಿಹಾರಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ.ಸಂ. | ಎಲ್.ಎ.ಸಿ. ಸಂಖ್ಯೆ | ಎಲ್‌ಎಸಿಎ ಸಂಖ್ಯೆ | ಕಲಮೂಡ ಗ್ರಾಮದ ಸ.ನಂ. | ವಿಸ್ತೀರ್ಣಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|---|
| 1 | 193/2006 | 35/2011 | 42/5 | 2–03 | 3,78,194–00 |
| | | | | ಒಟ್ಟು | **3,78,194–00** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 146 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ 19ನೇ ಜನವರಿ 2013.**

ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಕಲಮೂಡ ಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಕಲಮೂಡ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್ 42/5 ಜಮೀನಿಗೆ ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಮೊತ್ತ **ರೂ.3,78,194–00ಗಳನ್ನು** (ಮೂರು ಲಕ್ಷದ ಎಪ್ಪತ್ತೆಂಟು ಸಾವಿರದ ಒಂದುನೂರ ತೊಂಭತ್ನಾಲ್ಕು ರೂಪಾಯಿಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ **"**4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು**"** ಅಡಿಯಲ್ಲಿ ಒದಗಿಸಿರುವ ಅನುದಾನದಿಂದ **ರೂ.3,78,194–00/–ಗಳನ್ನು** ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ:20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR.209**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಗೋಗಿ ತಾಂಡ (ಕೆ) ಹತ್ತಿರ ಇಂಗು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2012–13/6140 ದಿನಾಂಕ 17/11/2012.

**ಪ್ರಸ್ತಾವನೆ:**

ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಗೋಗಿ ತಾಂಡ (ಕೆ) ಹತ್ತಿರ ಇಂಗು ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಗೋಗಿ ತಾಂಡಾದ(ಕೆ) ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 05/07/2007.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 19/02/2009.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಪಡೆದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಸಿವಿಲ್ ನ್ಯಾಯಾಲಯ(ಹಿರಿಯ ಶ್ರೇಣಿ) ಗುಲ್ಬರ್ಗಾ ಇಲ್ಲಿ ಎಲ್.ಎ.ಸಿ. ಪ್ರಕರಣ ಸಂಖ್ಯೆ:41/2010 ಮತ್ತು 42/2010ನ್ನು ದಾಖಲಿಸಿದ್ದು, ನ್ಯಾಯಾಲಯವು ದಿನಾಂಕ 16/01/2012ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ರೂ.1,37,000/–ಗಳನ್ನು ನಿಗದಿಪಡಿಸಿ ಆದೇಶಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಅಧಿಕಾರಿ–3(ಎಲ್.ಎ.ಸಿ) ಇವರ ಪತ್ರ ಸಂಖ್ಯೆ: ಆರ್‌ಡಿ 192 ಮತ್ತು 193 ಎಲ್‌ಸಿಜಿ 2012, ದಿನಾಂಕ 16/06/2012ರಂದು ಅಭಿಪ್ರಾಯ ನೀಡಿದೆ. ನ್ಯಾಯಾಲಯವು ಹೆಚ್ಚಿನ ಪರಿಹಾರಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ರೂ.3,59,657/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR.179**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ರಾಯಚೂರು ಜಿಲ್ಲೆ, ಸಿಂಧನೂರ ತಾಲ್ಲೂಕು ಹುಡಾ ಏತ ನೀರಾವರಿ ಯೋಜನೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011–12/4884, ದಿನಾಂಕ 21/09/2011.

**ಪ್ರಸ್ತಾವನೆ:**

ರಾಯಚೂರು ಜಿಲ್ಲೆ, ಸಿಂಧನೂರ ತಾಲ್ಲೂಕು ಹುಡಾ ಏತ ನೀರಾವರಿ ಕೆರೆ ಯೋಜನೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಮುಕ್ಕುಂದಾ ಮತ್ತು ಹುಡಾ ಗ್ರಾಮಗಳ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ದಿನಾಂಕ 21/09/2011ರ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 03/04/1997.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 15/03/2001.

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಭೂಮಾಲೀಕರು ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಲಿಂಗಸುಗೂರ ಸಿವಿಲ್ (ಹಿರಿಯ ವಿಭಾಗ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣಗಳನ್ನು ದಾಖಲಿಸಿದ್ದು, ನ್ಯಾಯಾಲಯವು ದಿನಾಂಕ 18/08/2007ರಂದು ನೀಡಿದ ಆದೇಶದಲ್ಲಿ ಎಲ್.ಎ.ಸಿ. ಸಂಖ್ಯೆ:262/2006ರಲ್ಲಿ ಪ್ರತಿ ಎಕರೆ ರೂ.86,400/–ಗಳನ್ನು, ಎಲ್.ಎ.ಸಿ. ಸಂಖ್ಯೆ:259/2006 ಮತ್ತು 260/2006ರಲ್ಲಿ ಪ್ರತಿ ಎಕರೆಗೆ ಜಮೀನಿಗೆ ರೂ.54,000/–ಗಳನ್ನು ನಿಗದಿಪಡಿಸಿ ಆದೇಶಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸಲು ಇದು ಅರ್ಹ ಪ್ರಕರಣವಲ್ಲವೆಂದು ಕಂದಾಯ ಇಲಾಖೆಯ ಕಾನೂನು ಅಧಿಕಾರಿ–III ಇವರು ಪತ್ರ ಸಂಖ್ಯೆ:ಆರ್‌ಡಿ 1285 ಎಲ್‌ಸಿಜಿ 2008, ದಿನಾಂಕ 04/02/2010ರಂದು ಅಭಿಪ್ರಾಯ ಪಟ್ಟಿದ್ದಾರೆ. ನ್ಯಾಯಾಲಯವು ಹೆಚ್ಚಿನ ಪರಿಹಾರಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ. ಸಂ. | ಎಲ್.ಎ.ಸಿ. ಸಂಖ್ಯೆ | ಸ.ನಂ. | ಗ್ರಾಮ | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|---|
| 1 | 259/2006 | 353/1 | ಮುಕ್ಕುಂದಾ | 0–21 | 130287 |
| 2 | 260/2006 | 216 | ಹುಡಾ | 0–04 | 9956 |
| 3 | 262/2006 | 183/ಬಿ | ಹುಡಾ | 0–08 | 29564 |
| | **ಒಟ್ಟು** | | | | **169807** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 149 ಭೂಸ್ವಾಪ್ರ 2011,ಬೆಂಗಳೂರು, ದಿನಾಂಕ 21ನೇ ಡಿಸೆಂಬರ್ 2012.**

ರಾಯಚೂರು ಜಿಲ್ಲೆ, ಸಿಂಧನೂರ ತಾಲ್ಲೂಕು ಹುಡಾ ಏತ ನೀರಾವರಿ ಯೋಜನೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಮುಕ್ಕುಂದಾ ಮತ್ತು ಹುಡಾ ಗ್ರಾಮಗಳಿಗೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನದ ಮೊತ್ತ ರೂ.1,69,807–00ಗಳನ್ನು (ಒಂದು ಲಕ್ಷದ ಅರವತ್ತೊಂಭತ್ತು ಸಾವಿರದ ಎಂಟುನೂರ ಏಳು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.

3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012-13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702-00-800-1-00-ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು-ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ರೂ.1,69,807/-ಗಳನ್ನು ಹಂಚಿಕೆ ಮಾಡಿ, ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/2010ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,

**ಕೆ.ಸಿ.ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR.180**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಗುಲ್ಬರ್ಗಾ ಜಿಲ್ಲೆ ಅಫ್‌ಜಲ್‌ಪುರ ತಾಲ್ಲೂಕು ಗೊಬ್ಬೂರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011-12/ 6629, ದಿನಾಂಕ 30/12/2011.

**ಪ್ರಸ್ತಾವನೆ:**

ಗುಲ್ಬರ್ಗಾ ಜಿಲ್ಲೆ ಅಫ್‌ಜಲ್‌ಪುರ ತಾಲ್ಲೂಕು ಗೊಬ್ಬೂರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಗೊಬ್ಬೂರ(ಕೆ) ಗ್ರಾಮದ ಜಮೀನುಗಳಿಗೆ ನ್ಯಾಯಾಲಯವು ನೀಡಿರುವ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 14/08/1997.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 05/11/1998.

ವಿಶೇಷ ಭೂಸ್ವಾಧೀನಾಧಿಕಾರಿಗಳು, ಗುಲ್ಬರ್ಗಾ ಇವರು ದಿನಾಂಕ 05/11/98ರಂದು ರಚಿಸಿದ ಐತೀರ್ಪಿನಂತೆ ಹಣ ಪಡೆದು, ಸ್ವಾಧೀನಕ್ಕೊಳಪಟ್ಟ ಗೊಬ್ಬೂರ(ಕೆ) ಗ್ರಾಮದ ಶ್ರೀ ಭೀಮಶ ಗಿರಿಮಲ್ಲಪ್ಪ ಎಂಬ ಭೂಮಾಲೀಕರು ಗುಲ್ಬರ್ಗಾ 2ನೇ ಹೆಚ್ಚುವರಿ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ಇವರು ಎಲ್.ಎ.ಸಿ. ಪ್ರಕರಣ ಸಂಖ್ಯೆ:536/99ನ್ನು ದಾಖಲಿಸಿದ್ದು, ನ್ಯಾಯಾಲಯವು ದಿನಾಂಕ 21/11/2002ರಂದು ನೀಡಿರುವ ಆದೇಶದಲ್ಲಿ ಪ್ರತಿ ಎಕರೆಗೆ ಒಣ ಭೂಮಿ ರೂ.36,200/-ಗಳು ಹಾಗೂ ಪೋಟಾಖರಾಬ್ ಜಮೀನಿಗೆ ರೂ.1,000/-ಗಳಿಗೆ ನಿಗದಿಪಡಿಸಿದೆ. ಈ ಆದೇಶಕ್ಕೆ ತೃಪ್ತರಾಗದ ಭೂಮಾಲೀಕರು ಉಚ್ಚ ನ್ಯಾಯಾಲಯದಲ್ಲಿ ಮೇಲ್ಮನವಿ ಎಂಎಫ್‌ಎ ಸಂಖ್ಯೆ:3700/04ನ್ನು ದಾಖಲಿಸಿದ್ದು, ಮಾನ್ಯ ನ್ಯಾಯಾಲಯವು ದಿನಾಂಕ 14/12/2005ರಂದು ನೀಡಲಾದ ಆದೇಶದಲ್ಲಿ ಭೂಮೌಲ್ಯವನ್ನು ರೂ.36,200/-ಗಳಿಂದ ರೂ.58,500/-ಗಳಿಗೆ ಹೆಚ್ಚಿಸಿದೆ.

ಉಚ್ಚ ನ್ಯಾಯಾಲಯದ ಆದೇಶವನ್ನು ಸಹ ಒಪ್ಪದ ಭೂಮಾಲೀಕರು ಮಾನ್ಯ ಸರ್ವೋಚ್ಚ ನ್ಯಾಯಾಲಯದಲ್ಲಿ ಮೇಲ್ಮನವಿ ಸಿವಿಲ್ ಅಪೀಲ್ 4742/08ನ್ನು ದಾಖಲಿಸಿದ್ದು, ಮಾನ್ಯ ಸರ್ವೋಚ್ಚ ನ್ಯಾಯಾಲಯವು ದಿನಾಂಕ 31/07/2008ರಂದು ನೀಡಲಾದ ಆದೇಶದಲ್ಲಿ ಪ್ರತಿ ಎಕರೆ ಜಮೀನಿಗೆ ರೂ.66,550/-ಗಳಿಗೆ ಹೆಚ್ಚಿಸಿ ಆದೇಶಿಸಿದೆ.

ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ ಸಂ | ಎಲ್‌ಎಸಿ | ಎಂಎಫ್‌ಎ | ಸಿ.ಎ. | ಗೊಬ್ಬೂರ(ಕೆ) ಗ್ರಾಮದ ಸ.ನಂ. | ವಿಸ್ತೀರ್ಣ ಎ-ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|---|---|
| 1 | 536/1999 | 3700/2004 | 4742/2008 | 24/3 & 24/4 | 7-10(ಒಣ) 0-25(ಪಿಕೆ) | 2,16,826-00 |
| | | | | | | **2,16,826-00** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 15 ಭೂಸ್ವಾಪ್ರ 2012,ಬೆಂಗಳೂರು, ದಿನಾಂಕ 28ನೇ ಡಿಸೆಂಬರ್ 2012.**

ಗುಲ್ಬರ್ಗಾ ಜಿಲ್ಲೆ, ಅಫ್‌ಜಲ್‌ಪುರ ತಾಲ್ಲೂಕು ಗೊಬ್ಬೂರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಗೊಬ್ಬೂರ(ಕೆ) ಗ್ರಾಮಕ್ಕೆ ಸೇರಿದ ಸರ್ವೆ ನಂಬರ್‌ಗಳ ಜಮೀನುಗಳಿಗೆ ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.2,16,826-ಗಳನ್ನು (ಎರಡು ಲಕ್ಷದ ಹದಿನಾರು ಸಾವಿರದ ಎಂಟುನೂರ ಇಪ್ಪತ್ತಾರು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ರೂ.2,16,826/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR.181**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಗುಲ್ಬರ್ಗಾ ಜಿಲ್ಲೆ, ಆಳಂದ ತಾಲ್ಲೂಕಿನ ಕೆರೂರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಭೂಸ್ವಾಧೀನ ಕಾಯ್ದೆ ಕಲಂ 28(ಎ)ರನ್ವಯ ವಿಶೇಷ ಭೂಸ್ವಾಧೀನಾಧಿಕಾರಿಗಳು, ಗುಲ್ಬರ್ಗಾ ಇವರ ಐತೀರ್ಪಿನಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 10/04/2012ರ ಪತ್ರ ಸಂಖ್ಯೆ:ಮುಇಂ/ಸನೀ (ಉ)ವ/ ಬಿಜಾ/ಭೂಸ್ವಾಪ್ರ/2011–12/2108.

**ಪ್ರಸ್ತಾವನೆ:**

ಗುಲ್ಬರ್ಗಾ ಜಿಲ್ಲೆ, ಆಳಂದ ತಾಲ್ಲೂಕಿನ ಕೆರೂರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಕೆರೂರ ಗ್ರಾಮದ ಜಮೀನುಗಳಿಗೆ ಭೂಸ್ವಾಧೀನ ಕಾಯ್ದೆ ಕಲಂ 28(ಎ)ರಡಿ ಪ್ರಕಾರ ವಿಶೇಷ ಭೂಸ್ವಾಧೀನಾಧಿಕಾರಿಗಳು, ಸಣ್ಣ ಮತ್ತು ಮಧ್ಯಮ ನೀರಾವರಿ ಯೋಜನೆಗಳು, ಗುಲ್ಬರ್ಗಾ ಇವರು ಹೊರಡಿಸಿರುವ ಐತೀರ್ಪಿನಂತೆ ಹೆಚ್ಚಿನ ಪರಿಹಾರ ಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ದಿನಾಂಕ 10/04/2012ರ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರು ಕೋರಿದ್ದಾರೆ. ಈ ಕೆರೆಯ ಭೂಸ್ವಾಧೀನ ಪ್ರಕ್ರಿಯೆಯ ವಿವರಗಳ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 18/12/1981
- ಭೂಸ್ವಾಧೀನಾಧಿಕಾರಿಗಳ ಮೂಲ ಐತೀರ್ಪಿನ ದಿನಾಂಕ 29/04/1983

ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳ ಕೆಲವೊಂದು ಭೂಮಾಲೀಕರು ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಗುಲ್ಬರ್ಗಾ ಸಿವಿಲ್ ನ್ಯಾಯಾಲಯ(ಹಿರಿಯ ವಿಭಾಗ)ದಲ್ಲಿ ದಾಖಲಿಸಿದ್ದ ಎಲ್.ಎ.ಸಿ. ಸಂಖ್ಯೆ:689/1995ರ ಪ್ರಕರಣದಲ್ಲಿ ಸಿವಿಲ್ ನ್ಯಾಯಾಲಯವು ದಿನಾಂಕ 09/07/1998ರಂದು ನೀಡಿರುವ ಆದೇಶದಲ್ಲಿ ಪ್ರತಿ ಎಕರೆಗೆ ರೂ.9,000/–ಗಳನ್ನು ನಿಗದಿಪಡಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಕೋಶವು ಪತ್ರ ಸಂಖ್ಯೆ:ಲಾ 421 ಎಲ್‌ಎಸ್‌ಜಿ 1998, ದಿನಾಂಕ 21/09/1998ರಲ್ಲಿ ಅಭಿಪ್ರಾಯ ನೀಡಿದೆ.

ಸಿವಿಲ್ ನ್ಯಾಯಾಲಯದ ತೀರ್ಪನ್ನು ಆಧರಿಸಿ ಭೂಸ್ವಾಧೀನದಲ್ಲಿ ಸೇರಿದ್ದ ಇತರೆ ಈ ಕೆಳಕಂಡ ಸ.ನಂ.ಗಳ ಭೂಮಾಲೀಕರು ಹೆಚ್ಚಿನ ಪರಿಹಾರ ಕೋರಿ ಸಲ್ಲಿಸಿದ ಅರ್ಜಿಯ ಮೇರೆಗೆ ವಿಶೇಷ ಭೂಸ್ವಾಧೀನಾಧಿಕಾರಿಗಳು, ಸಣ್ಣ ಮತ್ತು ಮಧ್ಯಮ ನೀರಾವರಿ ಯೋಜನೆಗಳು, ಗುಲ್ಬರ್ಗಾ ಇವರು ಭೂಸ್ವಾಧೀನ ಕಾಯ್ದೆ ಕಲಂ 28(ಎ)ರಡಿ ದಿನಾಂಕ 30/06/2009ರಂದು ಐತೀರ್ಪನ್ನು ರಚಿಸಿರುತ್ತಾರೆ.

| **ಭೂಸ್ವಾಧೀನ ಕಾಯ್ದೆ ಕಲಂ 28(ಎ)ರಡಿ ಐತೀರ್ಪಿನ ಸಂಖ್ಯೆ ಕಂ/ಭೂಸ್ವಾವಿ/1/29/1979–80ದಿನಾಂಕ 30/06/2009** | | | |
|---|---|---|---|
| **ಕ್ರ.ಸಂ.** | **ಒಕಳಿ ಗ್ರಾಮದ ಸ.ನಂ.** | **ವಿಸ್ತೀರ್ಣ ಎ–ಗುಂ** | **ಪರಿಹಾರ ಮೊತ್ತ (ರೂ.ಗಳಲ್ಲಿ)** |
| 1 | 8/1ಬಿ/1 | 2–12 | 1,06,607–00 |
| | **ಒಟ್ಟು** | | **1,06,607–00** |

ವಿಷಯವನ್ನು ಪರಿಶೀಲಿಸಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 75 ಭೂಸ್ವಾಪ್ರ 2012ಬೆಂಗಳೂರು, ದಿನಾಂಕ 05ನೇ ಜನವರಿ 2012.**

ಗುಲ್ಬರ್ಗಾ ಜಿಲ್ಲೆ, ಆಳಂದ ತಾಲ್ಲೂಕಿನ ಕೆರೂರ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಕೆರೂರ ಗ್ರಾಮದ ಜಮೀನುಗಳಿಗೆ ಭೂಸ್ವಾಧೀನ ಕಾಯ್ದೆ ಕಲಂ 28(ಎ) ಪ್ರಕಾರ ವಿಶೇಷ ಭೂಸ್ವಾಧೀನಾಧಿಕಾರಿಗಳು, ಗುಲ್ಬರ್ಗಾ ಇವರು ಹೊರಡಿಸಿರುವ ಐತೀರ್ಪಿನಂತೆ ಪರಿಹಾರ ಧನದ ಮೊತ್ತ ರೂ.1,06,607–00ಗಳನ್ನು(ಒಂದು ಲಕ್ಷದ ಆರು ಸಾವಿರದ ಆರುನೂರ ಏಳು ರೂ.ಗಳು ಮಾತ್ರ) ಪ್ರಸ್ತಾವನೆಯಲ್ಲಿ ತಿಳಿಸಿರುವ ಸ.ನಂ.ಗಳಿಗೆ ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ರೂ.1,06,607/–ಗಳನ್ನು ಹಂಚಿಕೆ ಮಾಡಿ, ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,

**ಕೆ.ಸಿ.ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

**PR.182** ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಧಾರವಾಡ ಜಿಲ್ಲೆ ಮತ್ತು ತಾಲ್ಲೂಕು ಹುಲಿಕೇರಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 31/10/2011ರ ಪತ್ರ ಸಂಖ್ಯೆ:ಮುಇಂ/ಸನೀ(ಉ)/ಭೂಸ್ವಾಪ್ರ/2011–12/5564.

**ಪ್ರಸ್ತಾವನೆ:**

ಧಾರವಾಡ ಜಿಲ್ಲೆ ಮತ್ತು ತಾಲ್ಲೂಕು ಹುಲಿಕೇರಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಹುಲಿಕೇರಿ ಗ್ರಾಮದ ಜಮೀನುಗಳಿಗೆ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣದಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ ಓದಲಾದ ದಿನಾಂಕ 31/10/2011ರ ಪತ್ರದಲ್ಲಿ ಕೋರಿದ್ದಾರೆ. ಹೆಚ್ಚಿನ ಪರಿಹಾರ ಧನಕ್ಕೆ ತೀರ್ಮ ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 20/12/1979
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಮ ಘೋಷಿಸಿದ ದಿನಾಂಕ 03/11/1982.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದ ಭೂಮಾಲೀಕರು ಹೆಚ್ಚಿನ ಪರಿಹಾರ ಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಧಾರವಾಡ ಹೆಚ್ಚುವರಿ ಸಿವಿಲ್ (ಹಿರಿಯ ವಿಭಾಗ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣ ಸಂಖ್ಯೆ:87/1997ನ್ನು ದಾಖಲಿಸಿದ್ದು, ನ್ಯಾಯಾಲಯವು ಪ್ರತಿ ಎಕರೆ ಜಮೀನಿಗೆ ರೂ.14,000/–ಗಳಂತೆ ನಿಗದಿಪಡಿಸಿ ಆದೇಶಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಕೋಶವು ಅಭಿಪ್ರಾಯ ನೀಡಿದೆ. ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ.ಸಂ. | ಎಲ್‌ಎಸಿ ಸಂಖ್ಯೆ | ಸ.ನಂ. | ಗ್ರಾಮ | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|---|
| 1 | 81/1997 | 34/1+2 | ಹುಲಿಕೇರಿ | 4–02 | 2,63,110–00 |
| | | | | **ಒಟ್ಟು** | **2,63,110–00** |

ಪ್ರಸ್ತಾವನೆಯನ್ನು ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 171 ಭೂಸ್ವಾಪ್ರ 2011,ಬೆಂಗಳೂರು, ದಿನಾಂಕ 28ನೇ ಡಿಸೆಂಬರ್ 2012.**

ಧಾರವಾಡ ಜಿಲ್ಲೆ ಮತ್ತು ತಾಲ್ಲೂಕು ಹುಲಿಕೇರಿ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಹುಲಿಕೇರಿ ಗ್ರಾಮಕ್ಕೆ ಸೇರಿದ 34/1+2ರ ಸರ್ವೆ ನಂಬರ್‌ನ ಜಮೀನಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣದಲ್ಲಿ ನೀಡಿರುವ ತೀರ್ಪಿನಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ

ರೂ.2,63,110–00ಗಳನ್ನು (ಎರಡು ಲಕ್ಷದ ಅರವತ್ತ್ಮೂರು ಸಾವಿರದ ಒಂದುನೂರ ಹತ್ತು ರೂ.ಗಳು ಮಾತ್ರ) ಪಾವತಿಸಲು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ರೂ.2,63,110/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR.184**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕಿನ ಪುರ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ದಿನಾಂಕ 02/07/2012ರ ಪತ್ರ ಸಂಖ್ಯೆ:ಮುಇಂ/ಸನೀ (ಉ)ವ/ ಬಿಜೆಪಿ/ಭೂಸ್ವಾಪ್ರ/2012–13/3839.

**ಪ್ರಸ್ತಾವನೆ:**

ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕಿನ ಪುರ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಕನ್ನಾಳ ಮತ್ತು ಸಂಗನಾಳ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ಮಾನ್ಯ ನ್ಯಾಯಾಲಯವು ನೀಡಿದ ತೀರ್ಪಿನಂತೆ ಹೆಚ್ಚಿನ ಪರಿಹಾರ ಧನ ಪಾವತಿಸಲು ರೂ.1,96,819–00ಗಳನ್ನು ಬಿಡುಗಡೆ ಮಾಡುವಂತೆ ಕೋರಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ ಓದಲಾದ ಪತ್ರದಲ್ಲಿ ಪ್ರಸ್ತಾವನೆ ಸಲ್ಲಿಸಿದ್ದಾರೆ. ಭೂಸ್ವಾಧೀನ ಪ್ರಕ್ರಿಯೆಯ ವಿವರಗಳು ಕೆಳಕಂಡಂತಿವೆ:

- ಭೂಸ್ವಾಧೀನ ಕಾಯ್ದೆ ಕಲಂ 4(1)ರ ಅಧಿಸೂಚನೆ ದಿನಾಂಕ 27/02/2003.
- ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ರಚಿಸಿದ ದಿನಾಂಕ 06/12/2005

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದ ಭೂಮಾಲೀಕರು ಹೆಚ್ಚಿನ ಪರಿಹಾರ ಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಕೊಪ್ಪಳ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣಗಳನ್ನು ದಾಖಲಿಸಿ ನ್ಯಾಯಾಲಯದಿಂದ ಹೆಚ್ಚಿನ ಪರಿಹಾರ ಧನಕ್ಕೆ ಆದೇಶ ಪಡೆದುಕೊಂಡಿದೆ. ನ್ಯಾಯಾಲಯದ ತೀರ್ಪಿನಲ್ಲಿ ಭೂಸ್ವಾಧೀನಾಧಿಕಾರಿಗಳು ಪ್ರತಿ ಎಕರೆಗೆ ನಿಗದಿಪಡಿಸಿದ್ದ ರೂ.12,000/–ಗಳಿಂದ ಪ್ರತಿ ಎಕರೆಗೆ ರೂ.1,08,000/–ಗಳಂತೆ ಹೆಚ್ಚಿಸಿ ಶಾಸನಬದ್ಧ ಇತರೆ ಸವಲತ್ತುಗಳನ್ನು ನೀಡಲು ಆದೇಶಿಸಲಾಗಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆ ಕಾನೂನು ಕೋಶವು ಪತ್ರ ಸಂಖ್ಯೆ:ಆರ್‌ಡಿ 619 ಎಲ್‌ಸಿಜಿ 2009, ದಿನಾಂಕ 21/05/2009ರಲ್ಲಿ ನಿರ್ಧಾರ ಕೈಗೊಂಡಿದೆ. ಅದರಂತೆ ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರ. ಸಂ | ಎಲ್‌ಎಸಿ ಸಂಖ್ಯೆ | ಸ.ನಂ. | ಗ್ರಾಮ | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 1 | 523/2008 | 31/1 | *ಕನ್ನಾಳ* | 0–11 | 94407 |
| 2 | 529/2008 | 16/1–2 | ಸಂಗನಾಳ | 0–12 | 102412 |
| | | | | **ಒಟ್ಟು** | **196819** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 108 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ 09ನೇ ಜನವರಿ 2013.**

ಕೊಪ್ಪಳ ಜಿಲ್ಲೆ, ಕುಷ್ಟಗಿ ತಾಲ್ಲೂಕಿನ ಪುರ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಕನ್ನಾಳ ಮತ್ತು ಸಂಗನಾಳ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಕೊಪ್ಪಳ (ಹಿರಿಯ ಶ್ರೇಣಿ) ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ಹಾಗೂ

ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.1,96,819/–ಗಳನ್ನು(ಒಂದು ಲಕ್ಷದ ತೊಂಭತ್ತಾರು ಸಾವಿರದ ಎಂಟುನೂರ ಹತ್ತೊಂಭತ್ತು ರೂ.ಗಳು ಮಾತ್ರ) ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ರೂ1,96,819/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರ ದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR.185**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ರಾಯಚೂರು ಜಿಲ್ಲೆ, ಲಿಂಗಸುಗೂರ ತಾಲ್ಲೂಕು ನಾಗಾಲಾಪೂರ ಗ್ರಾಮದ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2012–13/ 3837, ದಿನಾಂಕ 02/07/2012

**ಪ್ರಸ್ತಾವನೆ:**

ರಾಯಚೂರು ಜಿಲ್ಲೆ, ಲಿಂಗಸುಗೂರ ತಾಲ್ಲೂಕು ನಾಗಾಲಾಪೂರ ಗ್ರಾಮದ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಉಳಿಮೇಶ್ವರ ಮತ್ತು ಹಡಗಲಿ ಗ್ರಾಮಗಳ ಜಮೀನುಗಳ ಭೂಮಾಲೀಕರು ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಲಿಂಗಸೂಗೂರ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ದಾಖಲಿಸಿದ್ದ ಎಲ್.ಎ.ಸಿ. ಪ್ರಕರಣಗಳಲ್ಲಿ ಮಾನ್ಯ ನ್ಯಾಯಾಲಯವು ನೀಡಿದ ತೀರ್ಪಿನಂತೆ ಹೆಚ್ಚಿನ ಪರಿಹಾರ ಧನ ಪಾವತಿಸಲು ರೂ.15,11,449–00ಗಳನ್ನು ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 18/11/2004 .
- ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ರಚಿಸಿದ ದಿನಾಂಕ 29/11/2007. ಈ ಐತೀರ್ಪನ್ನು ಜಿಲ್ಲಾಧಿಕಾರಿಗಳು ದಿನಾಂಕ 29/12/2007ರಂದು ಅನುಮೋದಿಸಿದ್ದಾರೆ.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಧನ ಪಡೆದ ಭೂಮಾಲೀಕರು ಹೆಚ್ಚಿನ ಪರಿಹಾರ ಧನಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಲಿಂಗಸುಗೂರ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ದಾಖಲಿಸಿದ್ದ ಎಲ್.ಎ.ಸಿ. ಪ್ರಕರಣ ಸಂಖ್ಯೆ:17/2009 ರಿಂದ 21/2009ರ ಪ್ರಕರಣಗಳಲ್ಲಿ ನ್ಯಾಯಾಲಯವು ದಿನಾಂಕ 30/11/2010ರಂದು, ಎಲ್.ಎ.ಸಿ.ಸಂಖ್ಯೆ:22/2009ರ ಪ್ರಕರಣದಲ್ಲಿ ದಿನಾಂಕ 23/03/2011ರಂದು ಹಾಗೂ ಎಲ್.ಎ.ಸಿ.ಸಂಖ್ಯೆ:23/2009 ಮತ್ತು 24/2009ರ ಪ್ರಕರಣಗಳಲ್ಲಿ ದಿನಾಂಕ 20/04/2011ರಂದು ನೀಡಿದ ಆದೇಶಗಳಲ್ಲಿ ಪ್ರತಿ ಎಕರೆ ಜಮೀನಿಗೆ ರೂ.81,600/–ಗಳನ್ನು ನಿಗದಿಪಡಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಕೋಶವು ಪತ್ರ ಸಂಖ್ಯೆ:ಆರ್‌ಡಿ 413 ಎಲ್‌ಸಿಜಿ 2011, ದಿನಾಂಕ 24/11/2011, ಆರ್‌ಡಿ 526 ಎಲ್‌ಸಿಜಿ 2011, ಆರ್‌ಡಿ 527 ಎಲ್‌ಸಿಜಿ 2011 ಮತ್ತು ಆರ್‌ಡಿ 377 ಎಲ್‌ಸಿಜಿ 2011, ದಿನಾಂಕ 02/11/2012ರ ಪತ್ರಗಳಲ್ಲಿ ಅಭಿಪ್ರಾಯ ನೀಡಿದೆ.

ನ್ಯಾಯಾಲಯವು ಹೆಚ್ಚಿನ ಪರಿಹಾರಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ. ಸಂ | ಎಲ್‌ಎಸಿ ಸಂಖ್ಯೆ | ಸ.ನಂ. | ಗ್ರಾಮ | ವಿಸ್ತೀರ್ಣ ಎ–ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|---|
| 1 | 17/09 | 27/6 | ಉಳಿಮೇಶ್ವರ | 0–11 | 48702 |
| 2 | 18/09 | 25/2 | ಉಳಿಮೇಶ್ವರ | 1–04 | 193315 |
| 3 | 19/09 | 26/2 | ಉಳಿಮೇಶ್ವರ | 0–20 | 88143 |
| 4 | 20/09 | 27/4 | ಉಳಿಮೇಶ್ವರ | 0–14 | 61849 |
| 5 | 21/09 | 106/1 | ಹಡಗಲಿ | 3–00 | 526356 |
| 6 | 22/09 | 105/2 | ಹಡಗಲಿ | 2–00 | 351069 |
| 7 | 23/09 | 27/5 | ಉಳಿಮೇಶ್ವರ | 0–05 | 22409 |

| | | | | | |
|---|---|---|---|---|---|
| 8 | 24/09 | 23/2 | **ಉಳಿಮೇಶ್ವರ** | 1–10 | 219606 |
| | | | | **ಒಟ್ಟು** | **1511449** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 109 ಭೂಸ್ವಾಪ್ರ 2012,ಬೆಂಗಳೂರು, ದಿನಾಂಕ 18ನೇ ಜನವರಿ 2013.**

ರಾಯಚೂರು ಜಿಲ್ಲೆ, ಲಿಂಗಸುಗೂರ ತಾಲ್ಲೂಕು ನಾಗಾಲಾಪೂರ ಗ್ರಾಮದ ಬ್ರಿಡ್ಜ್ ಕಂ ಬ್ಯಾರೇಜ್ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಉಳಿಮೇಶ್ವರ ಮತ್ತು ಹಡಗಲಿ ಗ್ರಾಮಗಳಿಗೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣದಲ್ಲಿ ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಧನ ಮೊತ್ತ ರೂ.15,11,449–00ಗಳನ್ನು (ಹದಿನೈದು ಲಕ್ಷದ ಹನ್ನೊಂದು ಸಾವಿರದ ನಾನೂರ ನಲವತ್ತೊಂಭತ್ತು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ರೂ.15,11,449/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR.189**

## ಜಲ ಸಂಪನ್ಮೂಲ ಸಚಿವಾಲಯ

**ಸಂಖ್ಯೆ:ಸನೀಇ 106 ಭೂಸ್ವಾಪ್ರ 2012, ಬೆಂಗಳೂರು, ದಿನಾಂಕ 15–01–2013**

**ತಿದ್ದುಪಡಿ**

ಸರ್ಕಾರದ ಆದೇಶ ಸಂಖ್ಯೆ:ಸನೀಇ 106 ಭೂಸ್ವಾಪ್ರ 2012ರಲ್ಲಿ ನಮೂದಿಸಿರುವ ಸರ್ಕಾರದ ಆದೇಶದ **ದಿನಾಂಕ 05ನೇ ಜನವರಿ 2012** ಎಂಬುದರ ಬದಲಾಗಿ **ದಿನಾಂಕ 05ನೇ ಜನವರಿ 2013** ಎಂದು ತಿದ್ದಿ ಓದಿಕೊಳ್ಳತಕ್ಕದ್ದು.

ಉಳಿದಂತೆ ಯಾವುದೇ ಬದಲಾವಣೆ ಇರುವುದಿಲ್ಲ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR.191**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕು ನಾಗನೂರ ಗ್ರಾಮದ ಹದ್ದಿಯಲ್ಲಿ ಕೆರೆ ಕಾಲುವೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ರವರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2011–12/4887, ದಿನಾಂಕ 21/09/2011.

**ಪ್ರಸ್ತಾವನೆ:**

ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕು ನಾಗನೂರ ಗ್ರಾಮದ ಹದ್ದಿಯಲ್ಲಿ ಕೆರೆ ಕಾಲುವೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ನಾಗನೂರ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ದಿನಾಂಕ 21/09/2011ರ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಭೂಸ್ವಾಧೀನ ಪ್ರಕ್ರಿಯೆಯ ವಿವರಗಳು ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರ ಅಧಿಸೂಚನೆಯನ್ನು ದಿನಾಂಕ 03/06/1999ರಂದು ಹೊರಡಿಸಿದೆ.
- ಭೂಸ್ವಾಧೀನಾಧಿಕಾರಿಗಳು ಐತೀರ್ಪು ರಚಿಸಿದ ದಿನಾಂಕ 26/02/2001.

ಭೂಸ್ವಾಧೀನಾಧಿಕಾರಿಗಳು ರಚಿಸಿದ ಐತೀರ್ಪಿನಂತೆ ಹಣ ಪಡೆದು, ಹೆಚ್ಚಿನ ಪರಿಹಾರಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ರಾಮದುರ್ಗ ಸಿವಿಲ್ ನ್ಯಾಯಾಲಯ(ಹಿರಿಯ ವಿಭಾಗ)ದಲ್ಲಿ ಎಲ್.ಎ.ಸಿ. ಸಂಖ್ಯೆ:52/2007, 53/2007 ಮತ್ತು 54/2007ನ್ನು ದಾಖಲಿಸಿದ್ದು, ಸಿವಿಲ್ ನ್ಯಾಯಾಲಯ

ದಿನಾಂಕ 29/05/2008ರಂದು ನೀಡಿರುವ ಆದೇಶದಲ್ಲಿ ಪ್ರತಿ ಎಕರೆಗೆ ರೂ.1,04,000/–ಗಳ ಬೆಲೆಯನ್ನು ನಿಗದಿಪಡಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಅಧಿಕಾರಿ–III ಇವರು ಪತ್ರ ಸಂಖ್ಯೆ:ಆರ್‌ಡಿ 628 ಎಲ್‌ಸಿಬಿ 2008, ದಿನಾಂಕ 24/02/2010ರಂದು ಅಭಿಪ್ರಾಯ ಪಟ್ಟಿದ್ದಾರೆ. ಪಾವತಿಸಬೇಕಾದ ಪರಿಹಾರ ಮೊತ್ತದ ವಿವರ ಕೆಳಕಂಡಂತಿದೆ:

| ಕ್ರಸಂ. | ಎಲ್‌ಎಸಿ ಸಂಖ್ಯೆ | ನಾಗನೂರ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ–ಸೆಂ | ಪರಿಹಾರ ಮೊತ್ತ ರೂ.ಗಳಲ್ಲಿ |
|---|---|---|---|---|
| 1 | 52/2007 | 80 | 0–08–15 | 81592 |
| 2 | 53/2007 | 52/1ಎ | 0–04–15 | 48192 |
| 3 | 54/2007 | 61/1 | 0–19–00 | 188735 |
| | ಒಟ್ಟು | | | **318519** |

ಪ್ರಸ್ತಾವನೆಯಲ್ಲಿನ ಅಂಶಗಳನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು, ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 150 ಭೂಸ್ವಾಪ್ರ 2011,ಬೆಂಗಳೂರು, ದಿನಾಂಕ 11ನೇ ಡಿಸೆಂಬರ್ 2012.**

ಬೆಳಗಾಂ ಜಿಲ್ಲೆ, ರಾಮದುರ್ಗ ತಾಲ್ಲೂಕು ನಾಗನೂರ ಗ್ರಾಮದ ಹದ್ದಿಯಲ್ಲಿ ಕೆರೆ ಕಾಲುವೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ನಾಗನೂರ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್‌ಗಳ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿರುವ ತೀರ್ಪಿನಂತೆ ರೂ.3,18,519–00ಗಳನ್ನು (ಮೂರು ಲಕ್ಷದ ಹದಿನೆಂಟು ಸಾವಿರದ ಐನೂರ ಹತ್ತೊಂಭತ್ತು ರೂ.ಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ರೂ.3,18,519/–ಗಳನ್ನು ಹಂಚಿಕೆ ಮಾಡಿ, ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕ ಪ್ರತ್ಯಾಯೋಜನೆಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

PR.192

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಬೀದರ್ ಜಿಲ್ಲೆ ಮತ್ತು ತಾಲ್ಲೂಕಿನ ಅಷ್ಟೂರ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** 1) ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ವ್ಯವಹಾರದೊಂದಿಗೆ ಅಂತ್ಯಗೊಂಡಿರುವ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ ಭೂಸ್ವಾಪ್ರ/2012–13/6634, ದಿನಾಂಕ 10/12/2012.

2) ಕಾರ್ಯಪಾಲಕ ಇಂಜಿನಿಯರ್, ಸಣ್ಣ ನೀರಾವರಿ ವಿಭಾಗ, ಬೀದರ್ ಇವರ ಪತ್ರ ದಿನಾಂಕ 15/01/2013.

**ಪ್ರಸ್ತಾವನೆ:**

ಬೀದರ್ ಜಿಲ್ಲೆ ಮತ್ತು ತಾಲ್ಲೂಕಿನ ಅಷ್ಟೂರ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಮಿರ್ಜಾಪೂರ(ಟಿ) ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಕೋರಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಮೇಲೆ (1)ರಲ್ಲಿ ಓದಲಾದ ಪತ್ರದಲ್ಲಿ ಪ್ರಸ್ತಾವನೆ ಸಲ್ಲಿಸಿದ್ದಾರೆ. ಭೂಸ್ವಾಧೀನ ಪ್ರಕ್ರಿಯೆ ವಿವರಗಳು ಕೆಳಕಂಡಂತಿದೆ.

- ಭೂಸ್ವಾಧೀನ ಕಾಯ್ದೆ ಕಲಂ 4(1)ರ ಅಧಿಸೂಚನೆಯನ್ನು ದಿನಾಂಕ 15/07/2004 ರಂದು ಹೊರಡಿಸಲಾಗಿದೆ.
- ಭೂಸ್ವಾಧೀನಾಧಿಕಾರಿಗಳು ಐತೀರ್ಪು ರಚಿಸಿದ ದಿನಾಂಕ 30/06/2005.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಪಡೆದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಭೂಸ್ವಾಧೀನ ಕಾಯ್ದೆ ಕಲಂ 18(1)ರಡಿ ಬೀದರ್ ಸಿವಿಲ್ ಜಡ್ಜ್ (ಹಿರಿಯ ಶ್ರೇಣಿ) ನ್ಯಾಯಾಲಯದಲ್ಲಿ ಎಲ್.ಎ.ಸಿ. ಪ್ರಕರಣ ಸಂಖ್ಯೆ:8/06ನ್ನು ದಾಖಲಿಸಿದ್ದು, ಮಾನ್ಯ ನ್ಯಾಯಾಲಯವು ದಿನಾಂಕ 21/02/2009ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ಜಮೀನಿಗೆ ರೂ.4,35,600/–ಗಳನ್ನು ನಿಗದಿಪಡಿಸಿ ಇತರೆ ಸವಲತ್ತುಗಳೊಂದಿಗೆ ಪಾವತಿಸುವಂತೆ ಆದೇಶಿಸಿದೆ. ಈ ಆದೇಶದ ವಿರುದ್ಧ ವಿಶೇಷ ಭೂಸ್ವಾಧೀನಾಧಿಕಾರಿಗಳು, ಬೀದರ್ ಹಾಗೂ ಕಾರ್ಯಪಾಲಕ ಇಂಜಿನಿಯರ್, ಸಣ್ಣ ನೀರಾವರಿ ವಿಭಾಗ, ಬೀದರ್ ಇವರು ಮಾನ್ಯ ಉಚ್ಚ ನ್ಯಾಯಾಲಯದಲ್ಲಿ ಮೇಲ್ಮನವಿ ಎಂ.ಎಫ್.ಎ.ಸಂಖ್ಯೆ:30607/2011ನ್ನು ದಾಖಲಿಸಿದ್ದು, ಮಾನ್ಯ ನ್ಯಾಯಾಲಯವು ದಿನಾಂಕ 02/08/2011ರಂದು ನೀಡಿದ ಆದೇಶದಲ್ಲಿ ಮೇಲ್ಮನವಿಯನ್ನು ವಜಾಗೊಳಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಾನೂನು,

ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯು (ವ್ಯಾಜ್ಯಗಳು–7) ಅಭಿಪ್ರಾಯ ಪಟ್ಟಿದೆ. ಸದರಿ ಪ್ರಕರಣಕ್ಕೆ ಸಂಬಂಧಿಸಿದಂತೆ ಮಾನ್ಯ ಪ್ರಿನ್ಸಿಪಲ್ ಸಿವಿಲ್ ಜಡ್ಜ್ ನ್ಯಾಯಾಲಯ, ಬೀದರ್ ಇವರು ಬೀದರ್ ಸಣ್ಣ ನೀರಾವರಿ ವಿಭಾಗದ ಕಾರ್ಯಪಾಲಕ ಇಂಜಿನಿಯರ್‌ರವರಿಗೆ ಅರೆಸ್ಟ್ ವಾರೆಂಟ್ ಜಾರಿಗೊಳಿಸಲಾಗುವುದೆಂದು ನೋಟೀಸ್ ಜಾರಿ ಮಾಡಿರುವುದರಿಂದ, ಪರಿಹಾರ ಮೊತ್ತದ ಶೇ.50ರಷ್ಟು ಮೊತ್ತವನ್ನು ಬಿಡುಗಡೆ ಮಾಡಬೇಕೆಂದು ಕಾರ್ಯಪಾಲಕ ಇಂಜಿನಿಯರ್, ಸಣ್ಣ ನೀರಾವರಿ ವಿಭಾಗ, ಬೀದರ್ ಇವರು ಮೇಲೆ (2)ರಲ್ಲಿ ಓದಲಾದ ಪತ್ರದಲ್ಲಿ ಕೋರಿದ್ದಾರೆ. ಅದರಂತೆ ಪರಿಶೀಲಿಸಿ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 10 ಭೂಸ್ವಾಪ್ರ 2011,ಬೆಂಗಳೂರು, ದಿನಾಂಕ 19ನೇ ಜನವರಿ 2013.**

ಬೀದರ್ ಜಿಲ್ಲೆ ಮತ್ತು ತಾಲ್ಲೂಕಿನ ಅಷ್ಟೂರ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಂಡ ಮಿರ್ಜಾಪೂರ(ಟಿ) ಗ್ರಾಮದ ಜಮೀನುಗಳಿಗೆ ಸಿವಿಲ್ ನ್ಯಾಯಾಲಯವು ಎಲ್.ಎ.ಸಿ. ಪ್ರಕರಣದಲ್ಲಿ ನೀಡಿರುವ ತೀರ್ಪಿನಂತೆ ಪರಿಹಾರ ಮೊತ್ತದ ಶೇ.50ರಷ್ಟು ಅಂದರೆ ರೂ.67,02,671/–ಗಳನ್ನು (ಅರವತ್ತೇಳು ಲಕ್ಷದ ಎರಡು ಸಾವಿರದ ಆರುನೂರ ಎಪ್ಪತ್ತೊಂದು ರೂ.ಗಳು ಮಾತ್ರ) ಪಾವತಿಸಲು ಹಾಗೂ ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಸರ್ಕಾರವು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ರೂ.67,02,671/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ 20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕ ಪ್ರತ್ಯಾಯೋಜನೆ ಯನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,

**ಕೆ.ಸಿ.ಸಿದ್ದಪ್ಪ**

ಸರ್ಕಾರದ ಅಧೀನ ಕಾರ್ಯದರ್ಶಿ

ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR.193**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಓಕಳಿ ಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2012–13/5907 ದಿನಾಂಕ 31/10/2012.

**ಪ್ರಸ್ತಾವನೆ:**

ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಓಕಳಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಓಕಳಿ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 11/03/2004.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 01/07/2005.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಪಡೆದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಸಿವಿಲ್ ನ್ಯಾಯಾಲಯ(ಹಿರಿಯ ಶ್ರೇಣಿ) ಗುಲ್ಬರ್ಗಾ ಇಲ್ಲಿ ಎಲ್.ಎ.ಸಿ. ಪ್ರಕರಣ ಸಂಖ್ಯೆ:207/2006ನ್ನು ದಾಖಲಿಸಿದ್ದು, ನ್ಯಾಯಾಲಯವು ದಿನಾಂಕ 29/02/2007ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ರೂ.66,300/–ಗಳನ್ನು ನಿಗದಿಪಡಿಸಿ ಆದೇಶಿಸಿದೆ. ಸಿವಿಲ್ ನ್ಯಾಯಾಲಯದ ತೀರ್ಪಿಗೆ ತೃಪ್ತರಾಗದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಗುಲ್ಬರ್ಗಾ ಜಿಲ್ಲಾ ನ್ಯಾಯಾಲಯದಲ್ಲಿ ಮೇಲ್ಮನವಿ ಎಲ್.ಎ.ಸಿ.ಎ ಸಂಖ್ಯೆ:330/2010ಗಳನ್ನು ದಾಖಲಿಸಿದ್ದು, ಉಚ್ಚ ನ್ಯಾಯಾಲಯವು ದಿನಾಂಕ 19/11/2011ರಂದು ನೀಡಿದ ಆದೇಶದಲ್ಲಿ ರೂ.1,71,280/–ಗಳಿಗೆ ಹೆಚ್ಚಿಸಿ ಆದೇಶಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಅಧಿಕಾರಿ–3(ಎಲ್.ಎ.ಸಿ) ಇವರ ಪತ್ರ ಸಂಖ್ಯೆ: ಆರ್‌ಡಿ 24 ಎಲ್‌ಸಿಜಿ 2012, ದಿನಾಂಕ 16/06/2012ರಂದು ಅಭಿಪ್ರಾಯ ನೀಡಿದೆ. ನ್ಯಾಯಾಲಯವು ಹೆಚ್ಚಿನ ಪರಿಹಾರಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ ಸಂ. | ಎಲ್.ಎ.ಸಿ. ಸಂಖ್ಯೆ | ಎಲ್‌ಎಸಿಎ ಸಂಖ್ಯೆ | ಓಕಳಿ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|---|
| 1 | 207/2006 | 330/2010 | 55/1/1 | 2–11 | **5,75,279–00** |
| | **ಒಟ್ಟು** | | | | **5,75,279–00** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 152 ಭೂಸ್ವಾಪ್ರ 2012,ಬೆಂಗಳೂರು, ದಿನಾಂಕ: 19ನೇ ಜನವರಿ 2013.**

ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಓಕಳಿ ಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಓಕಳಿ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್ 55/1/1ರ ಜಮೀನಿಗೆ ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಮೊತ್ತ **ರೂ.5,75,279–00ಗಳನ್ನು** (ಐದು ಲಕ್ಷದ ಎಪ್ಪತ್ತೈದು ಸಾವಿರದ ಎರಡುನೂರ ಎಪ್ಪತ್ತೊಂಭತ್ತ ರೂಪಾಯಿಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ **ರೂ.5,75,279–00/–ಗಳನ್ನು** ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ:20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**P.R. 210**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಓಕಳಿ ಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2012–13/5644 ದಿನಾಂಕ 11/10/2012.

**ಪ್ರಸ್ತಾವನೆ:**

ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಓಕಳಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ವರನಾಳ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 23/06/2005.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 17/10/2006.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಪಡೆದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಸಿವಿಲ್ ನ್ಯಾಯಾಲಯ(ಹಿರಿಯ ಶ್ರೇಣಿ) ಗುಲ್ಬರ್ಗಾ ಇಲ್ಲಿ ಎಲ್.ಎ.ಸಿ. ಪ್ರಕರಣ ಸಂಖ್ಯೆ:103/07ನ್ನು ದಾಖಲಿಸಿದ್ದು, ನ್ಯಾಯಾಲಯವು ದಿನಾಂಕ 25/06/2010ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ರೂ.1,29,665/–ಗಳನ್ನು ನಿಗದಿಪಡಿಸಿ ಆದೇಶಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಅಧಿಕಾರಿ–3(ಎಲ್.ಎ.ಸಿ) ಇವರ ಪತ್ರ ಸಂಖ್ಯೆ: ಆರ್‌ಡಿ 933 ಎಲ್‌ಸಿಜಿ 2010, ದಿನಾಂಕ 28/05/2012ರಂದು ಅಭಿಪ್ರಾಯ ನೀಡಿದೆ. ನ್ಯಾಯಾಲಯವು ಹೆಚ್ಚಿನ ಪರಿಹಾರಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ ಸಂ. | ಎಲ್.ಎ.ಸಿ. ಸಂಖ್ಯೆ | ಓಕಳಿ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|
| 1 | 103/2007 | 55/5 | 2–20 | **7,88,463–00** |
| | | | | **7,88,463–00** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 156 ಭೂಸ್ವಾಪ್ರ 2012,ಬೆಂಗಳೂರು, ದಿನಾಂಕ: 19ನೇ ಜನವರಿ 2013.**

ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಓಕಳಿ ಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ವರನಾಳ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್ 55/5ರ ಜಮೀನಿಗೆ ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಮೊತ್ತ **ರೂ.7,88,463–00/–ಗಳನ್ನು** (ಏಳು ಲಕ್ಷದ ಎಂಭತ್ತೆಂಟು ಸಾವಿರದ ನಾಲ್ಕುನೂರ ಅರವತ್ತೂರು ರೂಪಾಯಿಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.

2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ರೂ.**7,88,463–00**/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ:20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**P.R. 212**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಭೂಯ್ಯಾರ ಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/2012–13/6338 ದಿನಾಂಕ 24/11/2012.

**ಪ್ರಸ್ತಾವನೆ:**

ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಭೂಯ್ಯಾರ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಅಂತಪನಾಳ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 13/01/1994.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 16/06/1995.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಪಡೆದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಸಿವಿಲ್ ನ್ಯಾಯಾಲಯ(ಹಿರಿಯ ಶ್ರೇಣಿ) ಗುಲ್ಬರ್ಗಾ ಇಲ್ಲಿ ಎಲ್.ಎ.ಸಿ. ಪ್ರಕರಣ ಸಂಖ್ಯೆ: 183/1998ನ್ನು ದಾಖಲಿಸಿದ್ದು, ಸಿವಿಲ್ ನ್ಯಾಯಾಲಯವು ದಿನಾಂಕ 25/11/2002ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ರೂ.30,000/–ಗಳನ್ನು ಒಣ ಭೂಮಿಗೆ ಹಾಗೂ ನೀರಾವರಿ ಜಮೀನಿಗೆ ರೂ.45,000/–ಗಳನ್ನು ನಿಗದಿಪಡಿಸಿ ಆದೇಶಿಸಿದೆ. ಸಿವಿಲ್ ನ್ಯಾಯಾಲಯದ ತೀರ್ಪಿಗೆ ತೃಪ್ತರಾಗದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಗುಲ್ಬರ್ಗಾ ಜಿಲ್ಲಾ ನ್ಯಾಯಾಲಯದಲ್ಲಿ ಮೇಲ್ಮನವಿ ಎಲ್.ಎ.ಸಿ.ಎ.ಪ್ರಕರಣ ಸಂಖ್ಯೆ: 328/2010ನ್ನು ದಾಖಲಿಸಿದ್ದು, ಜಿಲ್ಲಾ ನ್ಯಾಯಾಲಯವು ದಿನಾಂಕ 19/11/2011ರಂದು ನೀಡಿದ ಆದೇಶದಲ್ಲಿ ರೂ.74,700/–ಗಳನ್ನು ಒಣ ಭೂಮಿಗೆ ಹಾಗೂ ರೂ.1,12,350/–ಗಳನ್ನು ನೀರಾವರಿ ಜಮೀನಿಗೆ ಹೆಚ್ಚಿಸಿ ಆದೇಶಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಅಧಿಕಾರಿ–3(ಎಲ್.ಎ.ಸಿ) ಇವರ ಪತ್ರ ಸಂಖ್ಯೆ: ಆರ್‌ಡಿ 197 ಎಲ್‌ಸಿಜಿ 2012, ದಿನಾಂಕ 02/07/2012ರಂದು ಅಭಿಪ್ರಾಯ ನೀಡಿದೆ. ನ್ಯಾಯಾಲಯವು ಹೆಚ್ಚಿನ ಪರಿಹಾರಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ. ಸಂ. | ಎಲ್.ಎ.ಸಿ. ಸಂಖ್ಯೆ | ಎಲ್‌ಎಸಿಎ ಸಂಖ್ಯೆ | ಭೂಂಯಾರ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|---|
| 1 | 183/1998 | 328/2010 | 28/2 | 5–00(ಶಿ) | **18,57,817–00** |
| | | | | 3–20(ಆ) | |
| | | | | **ಒಟ್ಟು** | **18,57,817–00** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 158 ಭೂಸ್ವಾಪ್ರ 2012,ಬೆಂಗಳೂರು, ದಿನಾಂಕ 19ನೇ ಜನವರಿ 2013.**

ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಭೂಂಯಾರ ಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಅಂತಪನಾಳ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್ 28/2 ಜಮೀನಿಗೆ ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಮೊತ್ತ **ರೂ.18,57,817–00ಗಳನ್ನು (ಹದಿನೆಂಟು ಲಕ್ಷದ ಐವತ್ತೇಳು ಸಾವಿರದ ಎಂಟುನೂರ ಹದಿನೇಳು ರೂಪಾಯಿಗಳು ಮಾತ್ರ)** ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ **ರೂ.18,57,817/–ಗಳನ್ನು** ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ:20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**PR.219**

## ಜಲ ಸಂಪನ್ಮೂಲ ಸಚಿವಾಲಯ

**ವಿಷಯ:** ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಓಕಳಿ ಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರ ಪಾವತಿಸುವ ಬಗ್ಗೆ.

**ಓದಲಾಗಿದೆ:** ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರ ಪತ್ರ ಸಂಖ್ಯೆ:ಮುಇಂ/ಸನೀ(ಉ)ವ/ಬಿಜಾ/ಭೂಸ್ವಾಪ್ರ/ 2012–13/5645 ದಿನಾಂಕ 11/10/2012.

**ಪ್ರಸ್ತಾವನೆ:**

ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಓಕಳಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ವರನಾಳ ಗ್ರಾಮದ ಜಮೀನುಗಳಿಗೆ ಎಲ್.ಎ.ಸಿ. ಪ್ರಕರಣಗಳಲ್ಲಿ ನೀಡಿದ ತೀರ್ಪಿನ ಅನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ಅನುದಾನ ಬಿಡುಗಡೆ ಮಾಡುವಂತೆ ಮೇಲೆ ಓದಲಾದ ಪತ್ರದಲ್ಲಿ ಮುಖ್ಯ ಇಂಜಿನಿಯರ್, ಸಣ್ಣ ನೀರಾವರಿ ಉತ್ತರ ವಲಯ, ಬಿಜಾಪುರ ಇವರು ಕೋರಿದ್ದಾರೆ. ಹೆಚ್ಚಿನ ಪರಿಹಾರ ತೀರ್ಪು ನೀಡಿದ ಜಮೀನುಗಳ ಭೂಸ್ವಾಧೀನದ ಪ್ರಕ್ರಿಯೆಯ ವಿವರಗಳು ಈ ಕೆಳಕಂಡಂತಿದೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ 11/03/2004.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಭೂಸ್ವಾಧೀನಾಧಿಕಾರಿಗಳು ಪರಿಹಾರ ಧನದ ಐತೀರ್ಪು ಘೋಷಿಸಿದ ದಿನಾಂಕ 01/07/2005.

ಭೂಸ್ವಾಧೀನಾಧಿಕಾರಿಗಳ ಐತೀರ್ಪಿನಂತೆ ಪರಿಹಾರ ಪಡೆದ ಭೂಮಾಲೀಕರು ಇನ್ನೂ ಹೆಚ್ಚಿನ ಪರಿಹಾರಕ್ಕಾಗಿ ಸಿವಿಲ್ ನ್ಯಾಯಾಲಯ(ಹಿರಿಯ ಶ್ರೇಣಿ) ಗುಲ್ಬರ್ಗಾ ಇಲ್ಲಿ ಎಲ್.ಎ.ಸಿ. ಪ್ರಕರಣ ಸಂಖ್ಯೆ:210/2006ನ್ನು ದಾಖಲಿಸಿದ್ದು, ನ್ಯಾಯಾಲಯವು ದಿನಾಂಕ 25/06/2010ರಂದು ನೀಡಿದ ಆದೇಶದಲ್ಲಿ ಪ್ರತಿ ಎಕರೆ ರೂ.1,29,665/–ಗಳನ್ನು ನಿಗದಿಪಡಿಸಿ ಆದೇಶಿಸಿದೆ. ಈ ಆದೇಶದ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ಕಂದಾಯ ಇಲಾಖೆಯ ಕಾನೂನು ಅಧಿಕಾರಿ–3(ಎಲ್.ಎ.ಸಿ) ಇವರ ಪತ್ರ ಸಂಖ್ಯೆ: ಆರ್‌ಡಿ 944 ಎಲ್‌ಸಿಜಿ 2010, ದಿನಾಂಕ 28/05/2012ರಂದು ಅಭಿಪ್ರಾಯ ನೀಡಿದೆ. ನ್ಯಾಯಾಲಯವು ಹೆಚ್ಚಿನ ಪರಿಹಾರಕ್ಕೆ ತೀರ್ಪು ನೀಡಿರುವ ಪ್ರಕರಣಗಳ ವಿವರ ಕೆಳಕಂಡಂತಿದೆ:

| ಕ್ರ.ಸಂ. | ಎಲ್.ಎ.ಸಿ. ಸಂಖ್ಯೆ | ಓಕಳಿ ಗ್ರಾಮದ ಸ.ನಂ. | ವಿಸ್ತೀರ್ಣ ಎ–ಗುಂ | ಪರಿಹಾರ ಮೊತ್ತ (ರೂ.ಗಳಲ್ಲಿ) |
|---|---|---|---|---|
| 1 | 210/2006 | 55/4/7 | 2–22 | **8,49,006–00** |
| 2 | 211/2006 | 56 | 2–05 | **7,07,588–00** |
| | | | **ಒಟ್ಟು** | **15,56,594–00** |

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ:ಸನೀಇ 157 ಭೂಸ್ವಾಪ್ರ 2012,ಬೆಂಗಳೂರು, ದಿನಾಂಕ: 19ನೇ ಜನವರಿ 2013.**

ಗುಲ್ಬರ್ಗಾ ಜಿಲ್ಲೆ ಮತ್ತು ತಾಲ್ಲೂಕು ಓಕಳಿ ಕೆರೆಗಾಗಿ ಸ್ವಾಧೀನಪಡಿಸಿಕೊಳ್ಳಲಾದ ವರನಾಳ ಗ್ರಾಮಕ್ಕೆ ಸೇರಿದ ಮೇಲ್ಕಂಡ ಸರ್ವೆ ನಂಬರ್ 55/4/7 ಹಾಗೂ 56ರ ಜಮೀನುಗಳಿಗೆ ನ್ಯಾಯಾಲಯವು ನೀಡಿರುವ ತೀರ್ಪಿನಂತೆ ಹಾಗೂ ಭೂಸ್ವಾಧೀನ ಕಾಯ್ದೆಯಲ್ಲಿಯ ಸೂಚನೆಗಳಂತೆ ಲೆಕ್ಕಾಹಾಕಿದ ಪರಿಹಾರ ಮೊತ್ತ ರೂ.**15,56,594.00**/–ಗಳನ್ನು (ಹದಿನೈದು ಲಕ್ಷದ ಐವತ್ತಾರು ಸಾವಿರದ ಐದುನೂರ ತ್ತೊಂಭತ್ತಾಲ್ಕು ರೂಪಾಯಿಗಳು ಮಾತ್ರ) ಪಾವತಿಸಲು ಸರ್ಕಾರವು ಈ ಕೆಳಕಂಡ ಷರತ್ತುಗಳಿಗೊಳಪಟ್ಟು ಅನುಮೋದನೆ ನೀಡಿದೆ.

1. ಹಣ ಪಾವತಿಗೆ ಮೊದಲು ಮತ್ತೊಮ್ಮೆ ಲೆಕ್ಕಾಚಾರ ತ:ಖ್ತೆಯನ್ನು ದೃಢೀಕರಿಸಿಕೊಂಡು ಪಾವತಿಸತಕ್ಕದ್ದು ಹಾಗೂ ಎರಡನೇ ಬಾರಿ ಪಾವತಿಯಾಗದಂತೆ ಎಚ್ಚರವಹಿಸತಕ್ಕದ್ದು.
2. ಹೆಚ್ಚುವರಿ ಪರಿಹಾರಧನದ ಪಾವತಿಗೆ ಮೊದಲು ಜಮೀನಿನ ಹಕ್ಕುದಾರಿಕೆ ಬಗ್ಗೆ ಖಚಿತಪಡಿಸಿಕೊಂಡು ಪಾವತಿಸತಕ್ಕದ್ದು.
3. ಭೂಸ್ವಾಧೀನಕ್ಕೊಳಪಟ್ಟ ಜಮೀನುಗಳು ಇನ್ನೂ ಸಣ್ಣ ನೀರಾವರಿ ಇಲಾಖೆಯ ಹೆಸರಿಗೆ ವರ್ಗಾವಣೆಯಾಗದಿದ್ದಲ್ಲಿ, ಸಂಬಂಧಿಸಿದ ಸಹಾಯಕ ಕಾರ್ಯಪಾಲಕ ಇಂಜಿನಿಯರ್‌ರವರು ವರ್ಗಾವಣೆ ಬಗ್ಗೆ ಕೂಡಲೇ ಕ್ರಮ ಕೈಗೊಳ್ಳತಕ್ಕದ್ದು.

ಈ ವೆಚ್ಚವನ್ನು 2012–13ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ "4702–00–800–1–00–ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಂಗಳು–ಇತ್ಯರ್ಥ 132 ಬಂಡವಾಳ ವೆಚ್ಚಗಳು" ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ರೂ.**15,56,594.00**/–ಗಳನ್ನು ಹಂಚಿಕೆ ಮಾಡಿ ಬಿಡುಗಡೆ ಮಾಡಿದೆ.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂಖ್ಯೆ ಎಫ್‌ಡಿ 1 ಟಿಎಫ್‌ಪಿ 2010, ದಿನಾಂಕ:20/10/10ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರಮತ್ತು ಅವರ ಹೆಸರಿನಲ್ಲಿ,
**ಕೆ.ಸಿ.ಸಿದ್ದಪ್ಪ**
ಸರ್ಕಾರದ ಅಧೀನ ಕಾರ್ಯದರ್ಶಿ
ಜಲಸಂಪನ್ಮೂಲ ಇಲಾಖೆ(ಸಣ್ಣ ನೀರಾವರಿ)

**P.R. 220**

## ಒಳಾಡಳಿತ ಸಚಿವಾಲಯ

**ವಿಷಯ:** ನ್ಯಾಯಮೂರ್ತಿ ಶ್ರೀ ಆರ್.ಜಿ. ವೈದ್ಯನಾಥ ವಿಚಾರಣಾ ಆಯೋಗಕ್ಕೆ ಹಣ ಬಿಡುಗಡೆ ಮಾಡುವ ಬಗ್ಗೆ

**ಓದಲಾಗಿದೆ:**

1. ಅಧಿಸೂಚನೆ ಸಂಖ್ಯೆ:ಹೆಚ್‌ಡಿ 4 ಪಿಸಿಇ 2012 ದಿನಾಂಕ 09/03/2012.
2. ಸರ್ಕಾರದ ಆದೇಶ ಸಂಖ್ಯೆ:ಹೆಚ್‌ಡಿ 4 ಪಿಸಿಇ 2012 (ಭಾಗ–4) ದಿನಾಂಕ: 04/10/2012.
3. ಕಾರ್ಯದರ್ಶಿ, ನ್ಯಾಯಮೂರ್ತಿ ಶ್ರೀ ಆರ್.ಜಿ. ವೈದ್ಯನಾಥ ವಿಚಾರಣಾ ಆಯೋಗರವರ ಪತ್ರ ಸಂಖ್ಯೆ: ಆರ್‌ಜಿವಿಸಿ ನಂ.165/2012, ದಿನಾಂಕ: 18/12/2012.

**ಪ್ರಸ್ತಾವನೆ:**

ಮೇಲೆ (1)ರಲ್ಲಿ ಓದಲಾದ ಅಧಿಸೂಚನೆ ದಿನಾಂಕ:02/03/2012ರಂದು ಸಿಟಿ ಸಿವಿಲ್ ನ್ಯಾಯಾಲಯ, ಬೆಂಗಳೂರು ಇಲ್ಲಿ ವಕೀಲರು, ಮಾಧ್ಯಮ ಪ್ರತಿನಿಧಿಗಳು ಮತ್ತು ಪೊಲೀಸರ ನಡುವೆ ನಡೆದ ಘರ್ಷಣೆಯ ಕುರಿತು ಸತ್ಯಾಸತ್ಯತೆಯನ್ನು ತಿಳಿದುಕೊಳ್ಳಲು ನ್ಯಾಯಮೂರ್ತಿ ಶ್ರೀ ಆರ್.ಜಿ.ವೈದ್ಯನಾಥ, ನಿವೃತ್ತ ನ್ಯಾಯಾಧೀಶರು ಇವರ ನೇತೃತ್ವದಲ್ಲಿ ಏಕ ಸದಸ್ಯ ವಿಚಾರಣಾ ಆಯೋಗವನ್ನು ರಚಿಸಲಾಗಿದೆ. ಮೇಲೆ (2)ರಲ್ಲಿ ಓದಲಾದ ಸರ್ಕಾರಿ ಆದೇಶದಲ್ಲಿ ನ್ಯಾಯಮೂರ್ತಿ ಶ್ರೀ ಆರ್.ಜಿ.ವೈದ್ಯನಾಥ ವಿಚಾರಣಾ ಆಯೋಗದವರು ಸದರಿ ಆಯೋಗದ ಸಹಾಯಕ ಸಿಬ್ಬಂದಿಯ ವೇತನ ಪ್ರಾಸಂಗಿಕ ಖರ್ಚು–ವೆಚ್ಚ ಹಾಗೂ ಲೇಖನ ಸಾಮಗ್ರಿಗಳು ಮತ್ತು ಇತರೆ ಸಾಮಗ್ರಿಗಳನ್ನು ಖರೀದಿಸಲು ಅನುಕೂಲವಾಗುವಂತೆ ₹20,00,000/– (ರೂಪಾಯಿ ಇಪ್ಪತ್ತು ಲಕ್ಷಗಳು ಮಾತ್ರ)ಗಳನ್ನು ಬಿಡುಗಡೆ ಮಾಡಲಾಗಿತ್ತು. ಮೇಲೆ (3)ರಲ್ಲಿ ಓದಲಾದ ಪತ್ರದಲ್ಲಿ ಕಾರ್ಯದರ್ಶಿ ನ್ಯಾಯಮೂರ್ತಿ ಆರ್.ಜಿ. ವೈದ್ಯನಾಥ ವಿಚಾರಣಾ ಆಯೋಗ ಅವರು ಆಯೋಗವು ಮಾರ್ಚ್–2013ರವರೆಗೆ ಸಾಕ್ಷಿದಾರರಿಗೆ ಬಾಟ, ಪ್ರಯಾಣ ಭತ್ಯೆ ಮತ್ತು ನ್ಯಾಯಾಧೀಶರ ಕಾರ್ಯದರ್ಶಿ ಮತ್ತು ಸಿಬ್ಬಂದಿಯವರ ಸಂಬಳ, ವಕೀಲರ ಶುಲ್ಕ, ಲಾ ಬುಕ್‌ಗಳನ್ನು ಖರೀದಿಸಲು, ಕಂಪ್ಯೂಟರ್‌ಗಳ ರಿಪೇರಿ, ಇತರೆ ಪ್ರಾಸಂಗಿಕ ಖರ್ಚು–ವೆಚ್ಚಗಳಿಗಾಗಿ ಹೆಚ್ಚುವರಿ ₹25,00,000/– (ರೂಪಾಯಿ ಇಪ್ಪತ್ತೈದು ಲಕ್ಷಗಳು ಮಾತ್ರ)ಗಳನ್ನು ಬಿಡುಗಡೆ ಮಾಡುವಂತೆ ಸರ್ಕಾರವನ್ನು ಕೋರಿರುತ್ತಾರೆ. ಪ್ರಸ್ತಾವನೆಯನ್ನು ಸರ್ಕಾರವು ಕೂಲಂಕಷವಾಗಿ ಪರಿಶೀಲಿಸಿದೆ. ಆದ್ದರಿಂದ ಈ ಆದೇಶ.

**ಸರ್ಕಾರದ ಆದೇಶ ಸಂಖ್ಯೆ: ಹೆಚ್‌ಡಿ 4 ಪಿಸಿಇ 2012 (ಭಾಗ–4) ಬೆಂಗಳೂರು ದಿನಾಂಕ: 01/01/2013**

ನ್ಯಾಯಮೂರ್ತಿ ಶ್ರೀ ಆರ್.ಜಿ. ವೈದ್ಯನಾಥ, ವಿಚಾರಣಾ ಆಯೋಗಕ್ಕೆ ಸಹಾಯಕ ಸಿಬ್ಬಂದಿಯ ವೇತನ, ಪ್ರಾಸಂಗಿಕ ಖರ್ಚು–ವೆಚ್ಚ ಹಾಗೂ ಲೇಖನ ಸಾಮಗ್ರಿಗಳು ಮತ್ತು ಇತರೆ ಸಾಮಾಗ್ರಿಗಳನ್ನು ಖರೀದಿಸಲು ಅನುಕೂಲವಾಗುವಂತೆ 2012–2013ನೇ ಸಾಲಿಗೆ **₹10,00,000/– (ರೂಪಾಯಿ ಹತ್ತು ಲಕ್ಷಗಳು ಮಾತ್ರ)ಗಳನ್ನು ಲೆಕ್ಕ ಶೀರ್ಷಿಕೆ "2070–00–105–0–02–059 ಇತರ ವಿಚಾರಣಾ ಆಯೋಗ"** ಅಡಿಯಲ್ಲಿ ಭರಿಸುವಂತೆ ಹೆಚ್ಚುವರಿ ಅನುದಾನವನ್ನು ಸರ್ಕಾರವು ಬಿಡುಗಡೆ ಮಾಡಿದೆ.

ಸದರಿ ಆಯೋಗದ ಕಾರ್ಯದರ್ಶಿಯವರು ಹಣವನ್ನು ಹಿಂತೆಗೆಯುವ ಮತ್ತು ವಿತರಿಸುವ ಅಧಿಕಾರಿಯಾಗಿ ಕರ್ತವ್ಯ ನಿರ್ವಹಿಸುವರು.

ಸರ್ಕಾರದ ಆದೇಶ ಸಂಖ್ಯೆ:ಎಫ್‌ಡಿ 1 ಟಿಎಫ್‌ಪಿ 96 ದಿನಾಂಕ 10/07/1996ರಲ್ಲಿ ಸರ್ಕಾರದ ಪ್ರಧಾನ ಕಾರ್ಯದರ್ಶಿಗಳಿಗೆ ನೀಡಿರುವ ಅಧಿಕಾರ ಪ್ರತ್ಯಾಯೋಜನೆ ರೀತ್ಯಾ ಈ ಆದೇಶವನ್ನು ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಪ್ರಕಾಶ ವೈ.ಕೆ.**
ಸರ್ಕಾರದ ಅಧೀನ ಕಾರ್ಯದರ್ಶಿ,
ಒಳಾಡಳಿತ ಇಲಾಖೆ, (ಕಾನೂನು ಮತ್ತು ಸುವ್ಯವಸ್ಥೆ)

**P.R. 21**

## ಒಳಾಡಳಿತ ಸಚಿವಾಲಯ

**ವಿಷಯ:** ಶ್ರೀ ಎನ್.ಹೆಚ್. ರಾಜಶೇಖರ್, ಪಿ.ಎಸ್.ಐ., ದಾವಣಗೆರೆ, ಇವರು ಸರ್ಕಾರಕ್ಕೆ ಸಲ್ಲಿಸಿದ ಪರಿಷ್ಕರಣ ಮೇಲ್ಮನವಿ ಕುರಿತು ಅಂತಿಮ ಆದೇಶ.

**ಓದಲಾಗಿದೆ:**

1. ಶಿಸ್ತು ಪ್ರಾಧಿಕಾರ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಚಿತ್ರದುರ್ಗ, ಇವರ ಆದೇಶ ಸಂಖ್ಯೆ:ಸಿಬ್ಬಂದಿ(2) ಪಿಆರ್/124/10 (ಓ.ಬಿ. ಸಂಖ್ಯೆ: 279/11–12) ದಿನಾಂಕ: 12–10–2011.
2. ಮೇಲ್ಮನವಿ ಪ್ರಾಧಿಕಾರ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರ ಆದೇಶ ಸಂಖ್ಯೆ: 45/ಅಪೀಲು/ಸಿಬ್ಬಂದಿ–2/2011–12 (ಓಬಿ. ಸಂಖ್ಯೆ: 16/2012–13) ದಿನಾಂಕ:20–4–2012.
3. ಅರ್ಜಿದಾರರುಗಳ ಪರಿಷ್ಕರಣ ಮೇಲ್ಮನವಿ ಅರ್ಜಿ ದಿನಾಂಕ: 11–7–2012
4. ಮಹಾ ನಿರ್ದೇಶಕರು ಮತ್ತು ಆರಕ್ಷಕ ಮಹಾ ನಿರೀಕ್ಷಕರು, ಬೆಂಗಳೂರು, ಇವರ ಪತ್ರ ಸಂಖ್ಯೆ: ಅಪೀಲು(2)/21/2012/13 ದಿನಾಂಕ: 24–8–2012
5. ಕರ್ನಾಟಕ ಲೋಕಸೇವಾ ಆಯೋಗದ ಪತ್ರ ಸಂಖ್ಯೆ: ಪಿಎಸ್‌ಸಿ 123 ಸಿಐಎಸ್‌ಎಸ್ 2012 ದಿನಾಂಕ:07–11–2012

**ಪ್ರಸ್ತಾವನೆ:**

ಶ್ರೀ ಎನ್.ಹೆಚ್. ರಾಜಶೇಖರ್, ಇವರು ಭರಮಸಾಗರ ಪೊಲೀಸ್ ಠಾಣೆಯಲ್ಲಿ ಪಿ.ಎಸ್.ಐ. ಆಗಿ ಕರ್ತವ್ಯ ನಿರ್ವಹಿಸುತ್ತಿದ್ದಾಗ (ಇನ್ನು ಮುಂದೆ ಅರ್ಜಿದಾರರೆಂದು ಕರೆಯಲ್ಪಡುವ) ಕರ್ತವ್ಯದಲ್ಲಿ ಘೋರ ನಿರ್ಲಕ್ಷ್ಯತೆ ಮತ್ತು ಉದಾಸೀನತೆಯನ್ನು ಪ್ರದರ್ಶಿಸಿದ ಕಾರಣದ ಮೇಲೆ ಇವರ ವಿರುದ್ಧ ಕರ್ನಾಟಕ ರಾಜ್ಯ ಪೊಲೀಸ್ (ಶಿಸ್ತು ನಡವಳಿ) ನಿಯಮಗಳು 1965ರ ನಿಯಮ 7ರಡಿ ಈ ಕೆಳಕಂಡಂತೆ ದೋಷಾರೋಪಣೆಯನ್ನು ಹೊರಿಸಲಾಗಿದೆ.

**ದೋಷಾರೋಪಣೆ: –**

"ಶಿಸ್ತಿನ ಇಲಾಖೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿರುವ ಒಬ್ಬ ಜವಾಬ್ದಾರಿಯುತ ಪೊಲೀಸ್ ಅಧಿಕಾರಿಯಾಗಿ ಭರಮಸಾಗರ ಠಾಣೆ ಮೊ.ಸಂ. 215/08, ಸಿಸಿ.ನಂ. 1602/08ರಲ್ಲಿ ಪ್ರಕರಣದಲ್ಲಿ 1ನೇ ಜೆ.ಎಂ.ಎಫ್.ಸಿ. ನ್ಯಾಯಾಲಯ ಚಿತ್ರದುರ್ಗದಿಂದ 02 ಬಾರಿ ನೀಡಿದ ವಾರಂಟ್ಸ್‌ಗಳನ್ನು ಸಾಕ್ಷಿದಾರರುಗಳಿಗೆ ಜಾರಿ ಮಾಡಲು ವಿಫಲರಾಗಿ ಕರ್ತವ್ಯದಲ್ಲಿ ಘೋರ ನಿರ್ಲಕ್ಷತೆ ಮತ್ತು ಉದಾಸೀನತೆ ಪ್ರದರ್ಶಿಸಿದ ಬಗ್ಗೆ."

ಮೇಲ್ಕಂಡ ಆರೋಪದ ಮೇಲೆ ಅರ್ಜಿದಾರರ ಸಮಜಾಯಿಷಿ ಪಡೆದು ಅದನ್ನೊಪ್ಪದ ಶಿಸ್ತು ಪ್ರಾಧಿಕಾರಿ ಹಾಗೂ ಜಿಲ್ಲಾ ಪೊಲೀಸ್ ಅಧೀಕ್ಷಕರು, ಚಿತ್ರದುರ್ಗ, ಇವರು ಮೇಲೆ ಕ್ರಮ ಸಂಖ್ಯೆ: (1)ರಲ್ಲಿ ಓದಲಾದ ದಿನಾಂಕ: 12–10–2011ರ ಆದೇಶದಲ್ಲಿ ಅರ್ಜಿದಾರರ ಮುಂದಿನ ವಾರ್ಷಿಕ ವೇತನ ಬಡ್ತಿಯನ್ನು ಭವಿಷ್ಯದ ಬಡ್ತಿಗೆ ಪರಿಣಾಮ ಬೀರದಂತೆ ಒಂದು ವರ್ಷ ಕಾಲ ಮುಂದೂಡಲಾಗಿದೆ.

ಈ ಆದೇಶದ ವಿರುದ್ಧ ಸಲ್ಲಿಸಿದ ಅರ್ಜಿದಾರರ ಮೇಲ್ಮನವಿಯನ್ನು ಪರಿಶೀಲಿಸಿದ ಮೇಲ್ಮನವಿ ಪ್ರಾಧಿಕಾರಿ ಹಾಗೂ ಪೊಲೀಸ್ ಮಹಾ ನಿರೀಕ್ಷಕರು, ಪೂರ್ವ ವಲಯ, ದಾವಣಗೆರೆ, ಇವರು ಮೇಲೆ ಕ್ರಮ ಸಂಖ್ಯೆ: (2)ರಲ್ಲಿ ಓದಲಾದ ದಿನಾಂಕ: 20–4–2012ರ ಆದೇಶದಲ್ಲಿ ಮೇಲ್ಮನವಿಯನ್ನು ತಿರಸ್ಕರಿಸಿರುತ್ತಾರೆ.

ಈ ಎರಡೂ ಆದೇಶಗಳ ವಿರುದ್ಧ ಅರ್ಜಿದಾರರು ಸರ್ಕಾರಕ್ಕೆ ಪರಿಷ್ಕರಣ ಮೇಲ್ಮನವಿ ಅರ್ಜಿಯನ್ನು ಸಲ್ಲಿಸಿರುತ್ತಾರೆ. ಪರಿಷ್ಕರಣ ಮೇಲ್ಮನವಿ ಅರ್ಜಿಯಲ್ಲಿನ ವಾದಾಂಶಗಳನ್ನು ದಾಖಲೆಗಳೊಂದಿಗೆ ಪರಿಶೀಲಿಸಲಾಗಿದೆ. ಅರ್ಜಿದಾರರಿಗೆ ವಿಧಿಸಿದ ದಂಡನೆಯು ಆರೋಪಕ್ಕೆ ಅನುಗುಣವಾಗಿಲ್ಲವೆಂದು ಪರಿಗಣಿಸಿ, ಶಿಸ್ತು ಪ್ರಾಧಿಕಾರದ ದಂಡನಾದೇಶವನ್ನು ಭಾಗಶ: ಮಾರ್ಪಡಿಸುವ ಕುರಿತಂತೆ ಓದಲಾದ (5)ರ ಪತ್ರದಲ್ಲಿ ಕರ್ನಾಟಕ ಲೋಕಸೇವಾ ಆಯೋಗದ ಸಹಮತಿಯನ್ನು ಪಡೆದು ಸರ್ಕಾರವು ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಒಇ 73 ಪೊಸಿಅ 2012 ಬೆಂಗಳೂರು, ದಿನಾಂಕ: 08–11–2012**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳ ಹಿನ್ನೆಲೆಯಲ್ಲಿ, ಕರ್ನಾಟಕ ಪೊಲೀಸ್ ಅಧಿನಿಯಮ 1963ರ ಸೆಕ್ಷನ್ 25ರಡಿಯಲ್ಲಿ ಸರ್ಕಾರಕ್ಕೆ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಶ್ರೀ ಎನ್.ಹೆಚ್. ರಾಜಶೇಖರ್, ಪಿ.ಎಸ್.ಐ., ದಾವಣಗೆರೆ, ಇವರ ಪರಿಷ್ಕರಣ ಮೇಲ್ಮನವಿಯನ್ನು ಭಾಗಶ: ಪುರಸ್ಕರಿಸಿ ಶಿಸ್ತು ಪ್ರಾಧಿಕಾರದ ದಿನಾಂಕ: 12–10–2011ರ ಆದೇಶವನ್ನು ಮಾರ್ಪಡಿಸಿ ವಾಗ್ದಂಡನೆಯನ್ನು ವಿಧಿಸಿ ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ

**ಟಿ.ಎನ್. ರವಿಪ್ರಕಾಶ್,**

ಸರ್ಕಾರಿ ಅಧೀನ ಕಾರ್ಯದರ್ಶಿ,

ಒಳಾಡಳಿತ ಇಲಾಖೆ, (ಪೊಲೀಸ್ ಸೇವೆಗಳು)

**PR - 29**

## REVENUE SECRETARIAT

**Subject:-** Constitution of a High Level Committee under the Chairmanship of Chief Secretary to Government to monitor, protect and to prevent encroachment of Government lands – reg.

**READ :** Observations of the Hon'ble High Court of Karnataka in W.P.No.12249/2003 on 13-08-2012 and 17-08-2012.

**PREAMBLE :**

Government constituted a Joint Legislative Committee headed by Sri A.T. Ramaswamy, to study the encroachment of Government lands in and around Bangalore. The Committee submitted its report in two installments on 21-12-2006 and 12-07-2007 respectively.

2. A Task Force was also constituted on 19-09-2009 under the Charimanship fo Sri V. Balasubramanyam, Retired Additional Chief Secretary to study encroachments on government lands all over the state. The Task Force gave its report on 04-07-2011. To implement the recommendations of the Task Force, independent committees for Revenue, Forest and Urban Development Department were constituted under the charimanship of Departmental Secretaries.

3. The Karnataka Public Land Corporation Ltd was constituted on 28-08-2008, with an objective of preserving and protecting the Government lands besides preventing further encroachment.

4. To further consolidate the process of protection of Government lands, it is decided to constitute a High Level Committee headed by the Chief Secretary to Government. Hence, the following order.

**GOVERNMENT ORDER NO. RD 609 LGB 2012, BANGALORE DATED: 03-01-2013**

In the circumstances explained above, Government are pleased to constitute a High Level Committee to monitor the progress in eviction of encroachments and to protect the Government lands:-

| | | |
|---|---|---|
| 1. | The Chief Secretary to Government | Chairman |
| 2. | The Principal Secretary to Government, Revenue Department | Member |
| 3. | The Principal Secretary to Government, Finance Department | Member |

